RNI No. **KARBIL/2001/47147**

# ಕರ್ನಾಟಕ ರಾಜ್ಯಪತ್ರ

ಅಧಿಕೃತವಾಗಿ ಪ್ರಕಟಿಸಲಾದುದು

| ಸಂಪುಟ ೧೪೮<br>Volume 148 | ಬೆಂಗಳೂರು, ಗುರುವಾರ, ಏಪ್ರಿಲ್ ೧೧, ೨೦೧೩ (ಚೈತ್ರ ೨೧, ಶಕ ವರ್ಷ ೧೯೩೫)<br>Bangalore, Thursday, April 11, 2013 (Chaithra 21, Shaka Varsha 1935) | ಸಂಚಿಕೆ ೧೫<br>Issue 15 |
|---|---|---|

## ಭಾಗ ೧

## ರಾಜ್ಯ ಸರ್ಕಾರದ ಮುಖ್ಯ ಆದೇಶಗಳು ಹಾಗೂ ಸುತ್ತೋಲೆ ಮುಂತಾದ ಎಲ್ಲಾ ಇಲಾಖೆಗಳಿಗೂ ಸಂಬಂಧಿಸಿದ ಆದೇಶಗಳು

### ಜಲಸಂಪನ್ಮೂಲ ಸಚಿವಾಲಯ

**ವಿಷಯ :** ತುಮಕೂರು ಜಿಲ್ಲೆ, ಪಾವಗಡ ತಾಲ್ಲೂಕು, ಮರಿದಾನಹಳ್ಳಿ ವಸಂತನಕೆರೆ ಹೂಳೆತ್ತುವ ಕಾಮಗಾರಿಯ ಟೆಂಡರ್‌ನ ಅನುಮೋದನೆ ಬಗ್ಗೆ.

**ಓದಲಾಗಿದೆ :** ಮುಖ್ಯ ಇಂಜಿನಿಯರ್, ಸಣ್ಣ ನೀರಾವರಿ ದಕ್ಷಿಣ ವಲಯ ಬೆಂಗಳೂರುರವರ ಪತ್ರದ ಸಂಖ್ಯೆ : ಮುಸದ/ ತಾಂಸ-1-ಸ.ಇಂ-1/ತುಮಕೂರು/ಟೆಂಡರ್/2012-13/4346, ದಿನಾಂಕ : 15-12-2012.

**ಪ್ರಸ್ತಾವನೆ :**

ತುಮಕೂರು ಜಿಲ್ಲೆ, ಪಾವಗಡ ತಾಲ್ಲೂಕು, ಮರಿದಾನಹಳ್ಳಿ ವಸಂತನಕೆರೆ ಹೂಳೆತ್ತುವ ಕಾಮಗಾರಿಯ ರೂ. 10.00 ಲಕ್ಷಗಳ ಅಂದಾಜು ಪಟ್ಟಿಗೆ ಕಾರ್ಯಪಾಲಕ ಇಂಜಿನಿಯರ್, ಸಣ್ಣ ನೀರಾವರಿ ವಿಭಾಗ, ತುಮಕೂರು ಇವರು ಮಂಜೂರಾತಿ ನೀಡಿರುತ್ತಾರೆ.

ಈ ಕಾಮಗಾರಿಯನ್ನು ಕೈಗೊಳ್ಳಲು ತುಮಕೂರು ಸಣ್ಣ ನೀರಾವರಿ ವಿಭಾಗದಿಂದ ಕರೆಯಲಾದ ಟೆಂಡರ್‌ನ ಪ್ರಕಟಣೆಯನ್ನು ಕೆಳಕಂಡ ಮಾಧ್ಯಮಗಳಲ್ಲಿ ಪ್ರಕಟಿಸಲಾಗಿದೆ.

| | ಮೂಲ ಪ್ರಕಟಣೆ | ತಿದ್ದುಪಡಿ ಪ್ರಕಟಣೆ |
|---|---|---|
| ತುಮಕೂರು ಜಿಲ್ಲಾ ಟೆಂಡರ್ ಬುಲೆಟಿನ್ | 27-7-2012 | |
| ಪ್ರಜಾ ಪ್ರಗತಿ ದಿನ ಪತ್ರಿಕೆ | 29-7-2012 | 1-8-2012 |

ದಿನಾಂಕ 13-8-2012 ರಂದು ಇ-ಪ್ರೊಕ್ಯೂರ್‌ಮೆಂಟ್ ಮೂಲಕ ಟೆಂಡರ್ ಅನ್ನು ತೆರೆಯಲಾಗಿದ್ದು, ಈ ಟೆಂಡರ್ ಪ್ರಕಟಣೆಗೆ ಸ್ಪಂದಿಸಿ ನಾಲ್ಕು ಜನ ಗುತ್ತಿಗೆದಾರರು ಭಾಗವಹಿಸಿದ್ದು ಇವರಲ್ಲಿ ಒಬ್ಬರ ಟೆಂಡರ್ ಮಾತ್ರ ಅರ್ಹತೆ ಹೊಂದಿದ್ದು. ವಿವರಗಳು ಕೆಳಕಂಡಂತಿವೆ.

| ಮಂಜೂರಾದ ಅಂದಾಜಿನ ದರಗಳಂತೆ ಹಾಗೂ ಪ್ರಸಕ್ತ ಸಾಲಿನ ದರಗಳಿಗೆ ಪರಿಷ್ಕರಿಸಿದಂತೆ ಟೆಂಡರಿಗೆ ಇಡಲಾದ ಮೊತ್ತ | | | ರೂ. 9,94,816/- |
|---|---|---|---|
| ಕ್ರಮ ಸಂಖ್ಯೆ | ಗುತ್ತಿಗೆದಾರರ ಹೆಸರು ಮತ್ತು ದರ್ಜೆ ಶ್ರೀ/ಮೆಸರ್ಸ್ | ಟೆಂಡರ್‌ನಲ್ಲಿ ಗುತ್ತಿಗೆದಾರರು ನಮೂದಿಸಿರುವ ದರಗಳಂತೆ ಟೆಂಡರಿನ ಮೊತ್ತ | ಮಂಜೂರಾದ ಅಂದಾಜಿನ ದರಗಳ ಹಾಗೂ ಪ್ರಸಕ್ತ ಸಾಲಿನ ದರಗಳ ಮೇಲಿನ ಶೇಕಡಾವಾರು ಹೆಚ್ಚಳ/ಕಡಿಮೆ |
| 1. | ಕೆ.ಹೆಚ್. ರವೀಂದ್ರ, 1ನೇ ದರ್ಜೆ ಗುತ್ತಿಗೆದಾರರು | 10,89,889/- | 9.55 ಹೆಚ್ಚು |

ಮೇಲ್ಕಂಡಂತೆ ಶ್ರೀ ಕೆ.ಹೆಚ್. ರವೀಂದ್ರ, 1ನೇ ದರ್ಜೆ ಗುತ್ತಿಗೆದಾರರು ಇವರು ಟೆಂಡರ್‌ನಲ್ಲಿ ಅರ್ಹತೆ ಹೊಂದಿದ ಗುತ್ತಿಗೆದಾರರಾಗಿದ್ದು ಇವರು ನಮೂದಿಸಿದ ದರಗಳನ್ನು ಪ್ರಸಕ್ತ ಸಾಲಿನ ದರಗಳಿಗೆ ಪರಿಷ್ಕರಿಸಿದ ಟೆಂಡರ್‌ಗಿಟ್ಟ ಮೊತ್ತಕ್ಕೆ ಹೋಲಿಸಿದಾಗ ಶೇಕಡ 9.55 ರಷ್ಟು ಹೆಚ್ಚಾಗಿರುತ್ತದೆ. ಸದರಿ ಟೆಂಡರನ್ನು ಸರ್ಕಾರದಲ್ಲಿ ಪರಿಶೀಲಿಸಿ ಪರಿಷ್ಕೃತ ದರಗಳ ಮೇಲೆ ಶೇ. 9.50ರಷ್ಟು ಹೆಚ್ಚಿನ ದರಗಳಿಗೆ ಅಂದರೆ ರೂ. 10,89,324/- ಗಳಿಗೆ ಟೆಂಡರನ್ನು ಅನುಮೋದಿಸಲು ಪರಿಗಣಿಸಿದೆ.

ಮೇಲಿನ ಅಂಶಗಳ ಹಿನ್ನೆಲೆಯಲ್ಲಿ ಸರ್ಕಾರವು ಈ ಕೆಳಕಂಡಂತೆ ಆದೇಶ ಹೊರಡಿಸಿದೆ.

**ಸರ್ಕಾರದ ಆದೇಶ ಸಂಖ್ಯೆ : ಸನೀಇ 69 ಕೆಜಿದು 2012 (ತಾಂತ್ರಿಕ), ಬೆಂಗಳೂರು, ದಿನಾಂಕ : 15ನೇ ಜನವರಿ, 2013.**

ಪ್ರಸ್ತಾವನೆಯಲ್ಲಿ ವಿವರಿಸಿರುವ ಅಂಶಗಳ ಹಿನ್ನೆಲೆಯಲ್ಲಿ ತುಮಕೂರು ಜಿಲ್ಲೆ, ಪಾವಗಡ ತಾಲ್ಲೂಕು, ಮರಿದಾನಹಳ್ಳಿ ವಸಂತನಕೆರೆ ಹೂಳೆತ್ತುವ ಕಾಮಗಾರಿಯನ್ನು ಪ್ರಸಕ್ತ ಸಾಲಿನ ದರಪಟ್ಟಿಯ ದರಗಳನ್ನು ಪರಿಗಣಿಸಿ ಪರಿಷ್ಕರಿಸಿದಂತೆ ಟೆಂಡರಿಗಿಟ್ಟ ಮೊತ್ತ ರೂ. 9,94,816/–ಗಳ ಮೇಲೆ ಶೇ. 9.50 ರಷ್ಟು ಹೆಚ್ಚಿನ ದರದಲ್ಲಿ ಅಂದರೆ ರೂ. 10,89,324/–ಗಳಿಗೆ (ರೂ. ಹತ್ತು ಲಕ್ಷ ಎಂಬತ್ತು ಒಂಬತ್ತು ಸಾವಿರದ ಮೂರು ನೂರ ಇಪ್ಪತ್ತ ನಾಲ್ಕು ರೂಪಾಯಿಗಳು ಮಾತ್ರ) ಶ್ರೀ ಕೆ.ಹೆಚ್. ರವೀಂದ್ರ, 1ನೇ ದರ್ಜೆ ಗುತ್ತಿಗೆದಾರರಿಗೆ ಕೆಳಕಂಡ ಷರತ್ತುಗಳಿಗೆ ಒಳಪಡಿಸಿ ವಹಿಸಲು ಸರ್ಕಾರವು ಅನುಮೋದನೆ ನೀಡಿದೆ.

1. ಕಾಮಗಾರಿಯನ್ನು ನಿಗಧಿತ ಅವಧಿಯಲ್ಲಿ ಪೂರ್ಣಗೊಳಿಸತಕ್ಕದ್ದು.
2. ಸರ್ಕಾರದ ಅನುಮತಿ ಪಡೆಯದೆ ಕಾಮಗಾರಿಯಲ್ಲಿ ಯಾವುದೇ ಹೆಚ್ಚುವರಿ ಕೆಲಸ ನಿರ್ವಹಿಸಬಾರದು.

ಈ ಆದೇಶವನ್ನು ಆರ್ಥಿಕ ಇಲಾಖೆಯ ಆದೇಶ ಸಂಖ್ಯೆ : ಎಫ್‌ಡಿ 1 ಟಿಎಫ್‌ಪಿ 2002, ದಿನಾಂಕ: 20–1–2003 ರಲ್ಲಿ ಇಲಾಖಾ ಕಾರ್ಯದರ್ಶಿಯವರಿಗೆ ನೀಡಿರುವ ಆರ್ಥಿಕಾಧಿಕಾರದನ್ವಯ ಹೊರಡಿಸಲಾಗಿದೆ.

ಕರ್ನಾಟಕ ರಾಜ್ಯಪಾಲರ ಆದೇಶಾನುಸಾರ ಮತ್ತು ಅವರ ಹೆಸರಿನಲ್ಲಿ
**ರುದ್ರಮೂರ್ತಿ**
ಪದನಿಮಿತ್ತ ಸರ್ಕಾರದ ಅಧೀನ ಕಾರ್ಯದರ್ಶಿ,
ಜಲಸಂಪನ್ಮೂಲ ಇಲಾಖೆ (ಸಣ್ಣ ನೀರಾವರಿ).

**P.R. 122**

## ಜಲಸಂಪನ್ಮೂಲ ಸಚಿವಾಲಯ

**ವಿಷಯ :** ಹಾಸನ ಜಿಲ್ಲೆ , ಹಾಸನ ತಾಲ್ಲೂಕು (1) ಹಿರೇಕಡಲೂರು ಅಮಾನಿಕೆರೆ ಅಭಿವೃದ್ಧಿ (2) ಮೊಸಳೆ ದೊಡ್ಡಕೆರೆ ಅಭಿವೃದ್ಧಿ (3) ಕುದುರೆಗುಂಡಿ ದೊಡ್ಡಕೆರೆ ಅಭಿವೃದ್ಧಿ ಮತ್ತು (4) ಕಿತ್ತಾನೆಕೆರೆ ಅಭಿವೃದ್ಧಿ ಕಾಮಗಾರಿಗಳ ಪ್ಯಾಕೇಜ್ ಟೆಂಡರ್‌ಗೆ ಅನುಮೋದನೆ ನೀಡುವ ಬಗ್ಗೆ.

**ಓದಲಾಗಿದೆ :**
1. ಸರ್ಕಾರದ ಆದೇಶ ಸಂಖ್ಯೆ : ಸನೀಇ/03/ನಯೋಕಾ/2011, ದಿನಾಂಕ : 18–1–2012.
2. ಸರ್ಕಾರದ ಆದೇಶ ಸಂಖ್ಯೆ : ಸನೀಇ/03/ನಯೋಕಾ/2011, ದಿನಾಂಕ : 13–2–2012.
3. ಮುಖ್ಯ ಇಂಜಿನಿಯರ್, ಸಣ್ಣ ನೀರಾವರಿ ದಕ್ಷಿಣ ವಲಯ ಬೆಂಗಳೂರುರವರ ಪತ್ರದ ಸಂಖ್ಯೆ : ಮುಸದ/ತಾಂಸ–2/ಸ.ಇಂ–2/ನಬಾಡ್ ಆರ್.ಐ.ಡಿ.ಎಫ್–17/ಟೆಂಡರ್ ಇಂ.ನಂ. 4388/2012–13/3467, ದಿನಾಂಕ : 18–12–2012.

**ಪ್ರಸ್ತಾವನೆ :**

ಮೇಲೆ (1) ಮತ್ತು (2)ರಲ್ಲಿ ಓದಲಾದ ಸರ್ಕಾರದ ಆದೇಶಗಳಲ್ಲಿ ಆರ್.ಐ.ಡಿ.ಎಫ್–17 ರಡಿ ರೂ. 4172.82 ಲಕ್ಷ ಮೊತ್ತದ 178 ಕಾಮಗಾರಿಗಳ ಮತ್ತು ರೂ. 3478.03 ಲಕ್ಷ ಮೊತ್ತದ 111 ಕಾಮಗಾರಿಗಳ ಅಂದಾಜುಗಳಿಗೆ ನೀಡಲಾಗಿರುವ ಆಡಳಿತಾತ್ಮಕ ಅನುಮೋದನೆ ಕಾಮಗಾರಿಗಳ ಪೈಕಿ ಹಾಸನ ಜಿಲ್ಲೆ ಹಾಸನ ತಾಲ್ಲೂಕು (1) ಹಿರೇಕಡಲೂರು ಅಮಾನಿಕೆರೆ ಅಭಿವೃದ್ಧಿ (2) ಮೊಸಳೆ ದೊಡ್ಡಕೆರೆ ಅಭಿವೃದ್ಧಿ (3) ಕುದುರೆಗುಂಡಿ ದೊಡ್ಡಕೆರೆ ಅಭಿವೃದ್ಧಿ ಮತ್ತು (4) ಕಿತ್ತಾನೆಕೆರೆ ಅಭಿವೃದ್ಧಿ ಕಾಮಗಾರಿಗಳು ಇರುತ್ತವೆ. ಅಂದಾಜು ಪಟ್ಟಿಗಳಿಗೆ ಅಧೀಕ್ಷಕ ಇಂಜಿನಿಯರ್, ಸಣ್ಣ ನೀರಾವರಿ ವೃತ್ತ, ಮೈಸೂರು ಇವರು ಕೆಳಕಂಡಂತೆ ಮಂಜೂರಾತಿ ನೀಡಿರುತ್ತಾರೆ.

| | ಅಂದಾಜು ಮೊತ್ತ | ಸಿ.ಆರ್. ಸಂಖ್ಯೆ |
|---|---|---|
| 1. ಹಿರೇಕಡಲೂರು ಅಮಾನಿಕೆರೆ ಅಭಿವೃದ್ಧಿ | ರೂ. 40.00 ಲಕ್ಷ | 02/12–13 |
| 2. ಮೊಸಳೆ ದೊಡ್ಡಕೆರೆ ಅಭಿವೃದ್ಧಿ | ರೂ. 20.00 ಲಕ್ಷ | 179/11–12 |
| 3. ಕುದುರೆಗುಂಡಿ ದೊಡ್ಡಕೆರೆ ಅಭಿವೃದ್ಧಿ | ರೂ. 40.00 ಲಕ್ಷ | 03/11–12 |
| 4. ಕಿತ್ತಾನೆಕೆರೆ ಅಭಿವೃದ್ಧಿ | ರೂ. 50.00 ಲಕ್ಷ | 01/12–13 |
| **ಒಟ್ಟು** | **ರೂ. 150.00 ಲಕ್ಷ** | |

ಈ ಕಾಮಗಾರಿಯನ್ನು ಕೈಗೊಳ್ಳಲು ಹಾಸನ ಸಣ್ಣ ನೀರಾವರಿ ವಿಭಾಗದಿಂದ ಕರ್ನಾಟಕ ಸಾರ್ವಜನಿಕ ಸಂಗ್ರಹಣೆಗಳಲ್ಲಿ ಪಾರದರ್ಶಕತೆ ಅಧಿನಿಯಮದಡಿ ಇ–ಪ್ರೊಕ್ಯೂರ್‌ಮೆಂಟ್ ಮೂಲಕ ಕರೆಯಲಾದ ಟೆಂಡರ್ ಪ್ರಕಟಣೆಯನ್ನು ಕೆಳಕಂಡ ಮಾಧ್ಯಮಗಳಲ್ಲಿ ಪ್ರಕಟಿಸಲಾಗಿದೆ.

| | ಮೂಲ ಪ್ರಕಟಣೆ | ಮುಂದೂಡಿಕೆ ಪ್ರಕಟಣೆ |
|---|---|---|
| ರಾಜ್ಯ ಟೆಂಡರ್ ಬುಲೆಟಿನ್ | 28–8–2012 | |
| ಹಾಸನ ಜಿಲ್ಲಾ ಟೆಂಡರ್ ಬುಲೆಟಿನ್ | 25–8–2012 | 29–9–2012 |
| ವಿಜಯ ಕರ್ನಾಟಕ ದಿನ ಪತ್ರಿಕೆ | 25–8–2012 | 28–9–2012 |
| ವಾರ್ತಾ ಭಾರತಿ ದಿನ ಪತ್ರಿಕೆ | 26–8–2012 | |
| ಉದಯವಾಣಿ ದಿನ ಪತ್ರಿಕೆ | | 28–9–2012 |

ಈ ಟೆಂಡರ್ ಪ್ರಕಟಣೆಗೆ ಸ್ಪಂದಿಸಿ ಇಬ್ಬರು ಗುತ್ತಿಗೆದಾರರು ಬಿಡ್ ಅನ್ನು ಇ–ಪ್ರೊಕ್ಯೂರ್‌ಮೆಂಟ್ ಪೋರ್ಟಲ್‌ನಲ್ಲಿ ಅಪ್‌ಲೋಡ್ ಮಾಡಿರುತ್ತಾರೆ. ಇವರ ತಾಂತ್ರಿಕ ಬಿಡ್ ಅನ್ನು ದಿನಾಂಕ : 8–10–2012 ರಂದು ಇ–ಪ್ರೊಕ್ಯೂರ್‌ಮೆಂಟ್ ಮೂಲಕ ತೆರೆದು ಪರಿಶೀಲಿಸಲಾಗಿರುತ್ತದೆ. ಇವರಲ್ಲಿ ಒಬ್ಬರ ಬಿಡ್ ಮಾತ್ರ ಅರ್ಹತೆ ಹೊಂದಿದ್ದು, ಇವರ ಆರ್ಥಿಕ ಬಿಡ್ ಅನ್ನು ದಿನಾಂಕ : 31–10–2012 ರಂದು ತೆರೆಯಲಾಗಿದ್ದು ವಿವರಗಳು ಕೆಳಕಂಡಂತಿವೆ.

| ಮಂಜೂರಾದ ಅಂದಾಜಿನ ದರಗಳಂತೆ ಹಾಗೂ ಪ್ರಸಕ್ತ ಸಾಲಿನ ದರಗಳಿಗೆ ಪರಿಷ್ಕರಿಸಿದಂತೆ ಟೆಂಡರಿಗೆ ಇಡಲಾದ ಮೊತ್ತ | | | ರೂ. 148,81,644/– |
|---|---|---|---|
| ಕ್ರಮ ಸಂಖ್ಯೆ | ಗುತ್ತಿಗೆದಾರರ ಹೆಸರು ಮತ್ತು ದರ್ಜೆ ಶ್ರೀ/ಮೆಸರ್ಸ್ | ಟೆಂಡರ್‌ನಲ್ಲಿ ಗುತ್ತಿಗೆದಾರರು ನಮೂದಿಸಿರುವ ದರಗಳಂತೆ ಟೆಂಡರಿನ ಮೊತ್ತ | ಮಂಜೂರಾದ ಅಂದಾಜಿನ ದರಗಳ ಹಾಗೂ ಪ್ರಸಕ್ತ ಸಾಲಿನ ದರಗಳ ಮೇಲಿನ ಶೇಕಡಾವಾರು ಹೆಚ್ಚಳ/ಕಡಿಮೆ |
| 1. | ಎಸ್. ನಾರಾಯಣ ರೆಡ್ಡಿ, 1ನೇ ದರ್ಜೆ ಗುತ್ತಿಗೆದಾರರು | 171,50,441/– | 15.25 ಹೆಚ್ಚು |

ಮೇಲ್ಕಂಡಂತೆ ಶ್ರೀ ಎಸ್. ನಾರಾಯಣ ರೆಡ್ಡಿ, 1ನೇ ದರ್ಜೆ ಗುತ್ತಿಗೆದಾರರು ಇವರು ಟೆಂಡರ್‌ನಲ್ಲಿ ಅರ್ಹತೆ ಹೊಂದಿದ ಗುತ್ತಿಗೆದಾರರಾಗಿದ್ದು ಇವರು ನಮೂದಿಸಿದ ದರಗಳನ್ನು ಪ್ರಸಕ್ತ ಸಾಲಿನ ದರಗಳಿಗೆ ಪರಿಷ್ಕರಿಸಿದ ಟೆಂಡರ್‌ಗಿಟ್ಟ ಮೊತ್ತಕ್ಕೆ ಹೋಲಿಸಿದಾಗ ಶೇಕಡ 15.25 ರಷ್ಟು ಹೆಚ್ಚಾಗಿರುತ್ತದೆ. ಸದರಿ ಟೆಂಡರನ್ನು ಸರ್ಕಾರದಲ್ಲಿ ಪರಿಶೀಲಿಸಿ ಪರಿಷ್ಕೃತ ದರಗಳ ಮೇಲೆ ಶೇ. 13.00ರಷ್ಟು ಹೆಚ್ಚಿನ ದರಗಳಿಗೆ ಅಂದರೆ ರೂ. 168,16,258/– ಗಳಿಗೆ ಟೆಂಡರನ್ನು ಅನುಮೋದಿಸಲು ಪರಿಗಣಿಸಿದೆ.

ಮೇಲಿನ ಅಂಶಗಳ ಹಿನ್ನೆಲೆಯಲ್ಲಿ ಸರ್ಕಾರವು ಈ ಕೆಳಕಂಡಂತೆ ಆದೇಶ ಹೊರಡಿಸಿದೆ.

**ಸರ್ಕಾರದ ಆದೇಶ ಸಂಖ್ಯೆ : ಸನೀಇ 72 ಕೆಜಿದು 2012 (ತಾಂತ್ರಿಕ), ಬೆಂಗಳೂರು, ದಿನಾಂಕ : 8ನೇ ಜನವರಿ, 2013.**

ಪ್ರಸ್ತಾವನೆಯಲ್ಲಿ ವಿವರಿಸಿರುವ ಅಂಶಗಳ ಹಿನ್ನೆಲೆಯಲ್ಲಿ ಹಾಸನ ಜಿಲ್ಲೆ, ಹಾಸನ ತಾಲ್ಲೂಕು (1) ಹಿರೇಕಡಲೂರು ಅಮಾನಿಕೆರೆ ಅಭಿವೃದ್ಧಿ (2) ಮೊಸಳೆ ದೊಡ್ಡಕೆರೆ ಅಭಿವೃದ್ಧಿ (3) ಕುದುರೆಗುಂಡಿ ದೊಡ್ಡಕೆರೆ ಅಭಿವೃದ್ಧಿ ಮತ್ತು (4) ಕಿತ್ತಾನೆಕೆರೆ ಅಭಿವೃದ್ಧಿ ಕಾಮಗಾರಿಗಳನ್ನು ಪ್ರಸಕ್ತ ಸಾಲಿನ ದರಪಟ್ಟಿಯ ದರಗಳನ್ನು ಪರಿಗಣಿಸಿ ಪರಿಷ್ಕರಿಸಿದಂತೆ ಟೆಂಡರಿಗಿಟ್ಟ ಪರಿಷ್ಕೃತ ಮೊತ್ತ ರೂ. 148,81,644/–ಗಳ ಮೇಲೆ ಶೇ. 13.00ರಷ್ಟು ಹೆಚ್ಚಿನ ದರದಲ್ಲಿ ಅಂದರೆ ರೂ. 168,16,258/–ಗಳಿಗೆ (ರೂ. ಒಂದು ಕೋಟಿ ಅರವತ್ತ ಎಂಟು ಲಕ್ಷ ಹದಿನಾರು ಸಾವಿರದ ಎರಡು ನೂರ ಐವತ್ತೆಂಟು ರೂಪಾಯಿಗಳು ಮಾತ್ರ) ಶ್ರೀ ಎಸ್. ನಾರಾಯಣ ರೆಡ್ಡಿ, 1ನೇ ದರ್ಜೆ ಗುತ್ತಿಗೆದಾರರಿಗೆ ಕೆಳಕಂಡ ಷರತ್ತುಗಳಿಗೆ ಒಳಪಡಿಸಿ ವಹಿಸಲು ಸರ್ಕಾರವು ಅನುಮೋದನೆ ನೀಡಿದೆ.

1. ಕಾಮಗಾರಿಯನ್ನು ನಿಗಧಿತ ಅವಧಿಯಲ್ಲಿ ಪೂರ್ಣಗೊಳಿಸತಕ್ಕದ್ದು.
2. ಸರ್ಕಾರದ ಅನುಮತಿ ಪಡೆಯದೆ ಕಾಮಗಾರಿಯಲ್ಲಿ ಯಾವುದೇ ಹೆಚ್ಚುವರಿ ಕೆಲಸ ನಿರ್ವಹಿಸಬಾರದು.

ಈ ಆದೇಶವನ್ನು ಆರ್ಥಿಕ ಇಲಾಖೆಯ ಆದೇಶ ಸಂಖ್ಯೆ : ಎಫ್‌ಡಿ 1 ಟಿಎಫ್‌ಪಿ 2002, ದಿನಾಂಕ : 20–1–2003 ರಲ್ಲಿ ಇಲಾಖಾ ಕಾರ್ಯದರ್ಶಿಯವರಿಗೆ ನೀಡಿರುವ ಆರ್ಥಿಕಾಧಿಕಾರದನ್ವಯ ಹೊರಡಿಸಲಾಗಿದೆ.

ಕರ್ನಾಟಕ ರಾಜ್ಯಪಾಲರ ಆದೇಶಾನುಸಾರ ಮತ್ತು ಅವರ ಹೆಸರಿನಲ್ಲಿ

**ರುದ್ರಮೂರ್ತಿ**

ಪದನಿಮಿತ್ತ ಸರ್ಕಾರದ ಅಧೀನ ಕಾರ್ಯದರ್ಶಿ,

ಜಲಸಂಪನ್ಮೂಲ ಇಲಾಖೆ (ಸಣ್ಣ ನೀರಾವರಿ).

**P.R. 93**

## ಜಲಸಂಪನ್ಮೂಲ ಸಚಿವಾಲಯ

**ವಿಷಯ :** ಹಾಸನ ಜಿಲ್ಲೆ , ಹಾಸನ ತಾಲ್ಲೂಕು ಕೆಲವತ್ತಿ ಕೆರೆಯ ಅಭಿವೃದ್ಧಿ ಕಾಮಗಾರಿಯ ಟೆಂಡರ್ ಅನುಮೋದನೆ ಬಗ್ಗೆ.

**ಓದಲಾಗಿದೆ :**

1. ಸರ್ಕಾರದ ಆದೇಶ ಸಂಖ್ಯೆ : ಸನೀಇ 20 ಕೆಜಿದು (ತಾಂತ್ರಿಕ) 2011, ದಿನಾಂಕ : 8–6–2011
2. ಮುಖ್ಯ ಇಂಜಿನಿಯರ್, ಸಣ್ಣ ನೀರಾವರಿ ದಕ್ಷಿಣ ವಲಯ ಬೆಂಗಳೂರುರವರ ಪತ್ರದ ಸಂಖ್ಯೆ: ಮುಸದ/ತಾಂಸ–2/ಸ.ಇಂ–2/ಕೆಲವತ್ತಿಕೆರೆ/ಟೆಂಡರ್ ಇಂ.ನಂ. 4056 3ನೇ ಕರೆ/2012–13/4055, ದಿನಾಂಕ : 28–11–2012.

**ಪ್ರಸ್ತಾವನೆ :**

ಮೇಲೆ (1) ರಲ್ಲಿ ಓದಲಾದ ಸರ್ಕಾರದ ಆದೇಶಗಳಲ್ಲಿ "4702–ಕೆರೆಗಳ ಆಧುನೀಕರಣ (ಪ್ರಧಾನ ಕಾಮಗಾರಿಗಳು)" ಲೆಕ್ಕ ಶೀರ್ಷಿಕೆಯಡಿ ಹಾಸನ ಜಿಲ್ಲೆ, ಹಾಸನ ತಾಲ್ಲೂಕು, ಕೆಲವತ್ತಿ ಕೆರೆಯ ಅಭಿವೃದ್ಧಿ ಕಾಮಗಾರಿಯ ರೂ. 310.00 ಲಕ್ಷಗಳ ಅಂದಾಜು ಪಟ್ಟಿಗೆ ಆಡಳಿತಾತ್ಮಕ ಅನುಮೋದನೆ ನೀಡಿದ್ದು, ಮುಖ್ಯ ಇಂಜಿನಿಯರ್, ಸಣ್ಣ ನೀರಾವರಿ ದಕ್ಷಿಣ ವಲಯ, ಬೆಂಗಳೂರು ಇವರು ತಾಂತ್ರಿಕ ಮಂಜೂರಾತಿ ನೀಡಿರುತ್ತಾರೆ.

ಈ ಕಾಮಗಾರಿಯನ್ನು ಕೈಗೊಳ್ಳಲು ಹಾಸನ ಸಣ್ಣ ನೀರಾವರಿ ವಿಭಾಗದಿಂದ ಕರ್ನಾಟಕ ಸಾರ್ವಜನಿಕ ಸಂಗ್ರಹಣೆಗಳಲ್ಲಿ ಪಾರದರ್ಶಕತೆ ಅಧಿನಿಯಮದಡಿ ಇ–ಪ್ರೊಕ್ಯೂರ್‌ಮೆಂಟ್ ಮೂಲಕ 3ನೇ ಬಾರಿಗೆ ಕರೆಯಲಾದ ಟೆಂಡರ್ ಪ್ರಕಟಣೆಯನ್ನು ಕೆಳಕಂಡ ಮಾಧ್ಯಮಗಳಲ್ಲಿ ಪ್ರಕಟಿಸಲಾಗಿದೆ.

| | |
|---|---|
| ರಾಜ್ಯ ಟೆಂಡರ್ ಬುಲೆಟಿನ್ | 6–7–2012 |
| ಹಾಸನ ಜಿಲ್ಲಾ ಟೆಂಡರ್ ಬುಲೆಟಿನ್ | 7–7–2012 |
| ಪ್ರಜಾವಾಣಿ ದಿನ ಪತ್ರಿಕೆ | 9–7–2012 |
| ಹೊಸ ದಿಗಂತ ದಿನ ಪತ್ರಿಕೆ | 8–7–2012 |

ಈ ಟೆಂಡರ್ ಪ್ರಕಟಣೆಗೆ ಸ್ಪಂದಿಸಿ ಒಬ್ಬರು ಗುತ್ತಿಗೆದಾರರು ಮಾತ್ರ ಬಿಡ್ ಅನ್ನು ಇ-ಪ್ರೊಕ್ಯೂರ್‌ಮೆಂಟ್ ಪೋರ್ಟಲ್‌ನಲ್ಲಿ ಅಪ್‌ಲೋಡ್ ಮಾಡಿರುತ್ತಾರೆ. ಇವರ ತಾಂತ್ರಿಕ ಬಿಡ್ ಅನ್ನು ದಿನಾಂಕ : 15-9-2012 ರಂದು ಇ-ಪ್ರೊಕ್ಯೂರ್‌ಮೆಂಟ್ ಮೂಲಕ ತೆರೆದು ಪರಿಶೀಲಿಸಲಾಗಿರುತ್ತದೆ. ಇವರ ಬಿಡ್ ಅರ್ಹತೆ ಹೊಂದಿದ್ದು, ಇವರ ಆರ್ಥಿಕ ಬಿಡ್ ಅನ್ನು ದಿನಾಂಕ : 21-9-2012 ರಂದು ತೆರೆಯಲಾಗಿದ್ದು ವಿವರಗಳು ಕೆಳಕಂಡಂತಿವೆ.

| | | | | |
|---|---|---|---|---|
| ಮಂಜೂರಾದ ಅಂದಾಜಿನ ದರಗಳಂತೆ ಟೆಂಡರಿಗೆ ಇಡಲಾದ ಮೊತ್ತ | | | | ರೂ. 288,36,476/- |
| ಪ್ರಸಕ್ತ ಸಾಲಿನ ದರಪಟ್ಟಿಯ ದರಗಳಿಗೆ ಪರಿಷ್ಕರಿಸಿದಂತೆ ಟೆಂಡರಿಗೆ ಇಡಲಾದ ಮೊತ್ತ | | | | ರೂ. 288,94,408/- |
| ಕ್ರಮ ಸಂಖ್ಯೆ | ಗುತ್ತಿಗೆದಾರರ ಹೆಸರು ಮತ್ತು ದರ್ಜೆ ಶ್ರೀ/ಮೆಸರ್ಸ್ | ಟೆಂಡರ್‌ನಲ್ಲಿ ಗುತ್ತಿಗೆದಾರರು ನಮೂದಿಸಿರುವ ದರಗಳಂತೆ ಟೆಂಡರಿನ ಮೊತ್ತ | ಮಂಜೂರಾದ ಅಂದಾಜಿನ ದರಗಳ ಮೇಲಿನ ಶೇಕಡಾವಾರು ಹೆಚ್ಚಳ/ಕಡಿಮೆ | ಪರಿಷ್ಕರಿಸಿದ ದರಗಳ ಮೇಲಿನ ಶೇಕಡಾವಾರು ಹೆಚ್ಚಳ/ಕಡಿಮೆ |
| 1. | ಬಿ.ಎಸ್. ಅಶೋಕ್, 1ನೇ ದರ್ಜೆ ಗುತ್ತಿಗೆದಾರರು | 340,69,027/- | 18.15 ಹೆಚ್ಚು | 17.91 ಹೆಚ್ಚು |

ಮೇಲ್ಕಂಡಂತೆ ಶ್ರೀ ಬಿ.ಎಸ್. ಅಶೋಕ್, 1ನೇ ದರ್ಜೆ ಗುತ್ತಿಗೆದಾರರು ಇವರು ಟೆಂಡರ್‌ನಲ್ಲಿ ಅರ್ಹತೆ ಹೊಂದಿದ ಗುತ್ತಿಗೆದಾರರಾಗಿದ್ದು ಇವರು ನಮೂದಿಸಿದ ದರಗಳನ್ನು ಪ್ರಸಕ್ತ ಸಾಲಿನ ದರಗಳಿಗೆ ಪರಿಷ್ಕರಿಸಿದ ಟೆಂಡರ್‌ಗಿಟ್ಟ ಮೊತ್ತಕ್ಕೆ ಹೋಲಿಸಿದಾಗ ಶೇಕಡ 17.91 ರಷ್ಟು ಹೆಚ್ಚಾಗಿರುತ್ತದೆ. ಸದರಿ ಟೆಂಡರನ್ನು ಪರಿಶೀಲಿಸಿ ಪರಿಷ್ಕೃತ ದರಗಳ ಮೇಲೆ ಶೇ. 13.00ರಷ್ಟು ಹೆಚ್ಚಿನ ದರಗಳಿಗೆ ಅಂದರೆ ರೂ. 326,50,681/- ಗಳಿಗೆ ಟೆಂಡರನ್ನು ಅನುಮೋದಿಸಲು ಪರಿಗಣಿಸಿದೆ.

ಮೇಲಿನ ಅಂಶಗಳ ಹಿನ್ನೆಲೆಯಲ್ಲಿ ಸರ್ಕಾರವು ಈ ಕೆಳಕಂಡಂತೆ ಆದೇಶ ಹೊರಡಿಸಿದೆ.

**ಸರ್ಕಾರದ ಆದೇಶ ಸಂಖ್ಯೆ : ಸನೀಇ 66 ಕೆಜಿದು 2012 (ತಾಂತ್ರಿಕ), ಬೆಂಗಳೂರು, ದಿನಾಂಕ : 8ನೇ ಜನವರಿ, 2013.**

ಪ್ರಸ್ತಾವನೆಯಲ್ಲಿ ವಿವರಿಸಿರುವ ಅಂಶಗಳ ಹಿನ್ನೆಲೆಯಲ್ಲಿ ಹಾಸನ ಜಿಲ್ಲೆ , ಹಾಸನ ತಾಲ್ಲೂಕು ಕೆಲವತ್ತಿ ಕೆರೆಯ ಅಭಿವೃದ್ಧಿ ಕಾಮಗಾರಿಗಳನ್ನು ಪ್ರಸಕ್ತ ಸಾಲಿನ ದರಪಟ್ಟಿಯ ದರಗಳನ್ನು ಪರಿಗಣಿಸಿ ಪರಿಷ್ಕರಿಸಿದಂತೆ ಟೆಂಡರಿಗಿಟ್ಟ ಪರಿಷ್ಕೃತ ಮೊತ್ತ ರೂ. 288,94,408/-ಗಳ ಮೇಲೆ ಶೇ. 13.00 ರಷ್ಟು ಹೆಚ್ಚಿನ ದರದಲ್ಲಿ ಅಂದರೆ ರೂ. 326,50,681/-ಗಳಿಗೆ (ರೂ. ಮೂರು ಕೋಟಿ ಇಪ್ಪತ್ತ ಆರು ಲಕ್ಷ ಐವತ್ತು ಸಾವಿರದ ಆರು ನೂರ ಎಂಬತ್ತ ಒಂದು ರೂಪಾಯಿಗಳು ಮಾತ್ರ) ಕಾಮಗಾರಿಯನ್ನು ಶ್ರೀ ಬಿ.ಎಸ್. ಅಶೋಕ್, 1ನೇ ದರ್ಜೆ ಗುತ್ತಿಗೆದಾರರಿಗೆ ಕೆಳಕಂಡ ಷರತ್ತುಗಳಿಗೆ ಒಳಪಡಿಸಿ ವಹಿಸಲು ಸರ್ಕಾರವು ಅನುಮೋದನೆ ನೀಡಿದೆ.

1. ಕಾಮಗಾರಿಯನ್ನು ನಿಗಧಿತ ಅವಧಿಯಲ್ಲಿ ಪೂರ್ಣಗೊಳಿಸತಕ್ಕದ್ದು.
2. ಸರ್ಕಾರದ ಅನುಮತಿ ಪಡೆಯದೆ ಕಾಮಗಾರಿಯಲ್ಲಿ ಯಾವುದೇ ಹೆಚ್ಚುವರಿ ಕೆಲಸ ನಿರ್ವಹಿಸಬಾರದು.

ಈ ಆದೇಶವನ್ನು ಆರ್ಥಿಕ ಇಲಾಖೆಯ ಆದೇಶ ಸಂಖ್ಯೆ : ಎಫ್‌ಡಿ 1 ಟಿಎಫ್‌ಪಿ 2002, ದಿನಾಂಕ : 20-1-2003 ರಲ್ಲಿ ಇಲಾಖಾ ಕಾರ್ಯದರ್ಶಿಯವರಿಗೆ ನೀಡಿರುವ ಆರ್ಥಿಕಾಧಿಕಾರದನ್ವಯ ಹೊರಡಿಸಲಾಗಿದೆ.

ಕರ್ನಾಟಕ ರಾಜ್ಯಪಾಲರ ಆದೇಶಾನುಸಾರ ಮತ್ತು ಅವರ ಹೆಸರಿನಲ್ಲಿ
**ರುದ್ರಮೂರ್ತಿ**
ಪದನಿಮಿತ್ತ ಸರ್ಕಾರದ ಅಧೀನ ಕಾರ್ಯದರ್ಶಿ,
ಜಲಸಂಪನ್ಮೂಲ ಇಲಾಖೆ (ಸಣ್ಣ ನೀರಾವರಿ).

**P.R. 95**

## ಜಲಸಂಪನ್ಮೂಲ ಸಚಿವಾಲಯ

**ವಿಷಯ :** ತುಮಕೂರು ಜಿಲ್ಲೆ, ಪಾವಗಡ ತಾಲ್ಲೂಕು, ತಿರುಮಣಿ ಕೆರೆ ಹೂಳೆತ್ತುವ ಕಾಮಗಾರಿಯ ಟೆಂಡರ್‌ನ ಅನುಮೋದನೆ ಬಗ್ಗೆ.

**ಓದಲಾಗಿದೆ :** ಮುಖ್ಯ ಇಂಜಿನಿಯರ್, ಸಣ್ಣ ನೀರಾವರಿ ದಕ್ಷಿಣ ವಲಯ ಬೆಂಗಳೂರುರವರ ಪತ್ರದ ಸಂಖ್ಯೆ : ಮುಸದ/ತಾಂಸ-1/ಸ.ಇಂ-1/ತುಮಕೂರು/ಟೆಂಡರ್/2012-13/3943, ದಿನಾಂಕ : 22-11-2012.

**ಪ್ರಸ್ತಾವನೆ :**

ತುಮಕೂರು ಜಿಲ್ಲೆ, ಪಾವಗಡ ತಾಲ್ಲೂಕು, ತಿರುಮಣಿ ಕೆರೆ ಹೂಳೆತ್ತುವ ಕಾಮಗಾರಿಯ ರೂ. 10.00 ಲಕ್ಷಗಳ ಅಂದಾಜು ಪಟ್ಟಿಗೆ ಕಾರ್ಯಪಾಲಕ ಇಂಜಿನಿಯರ್, ಸಣ್ಣ ನೀರಾವರಿ ವಿಭಾಗ, ತುಮಕೂರು ಇವರು ಮಂಜೂರಾತಿ ನೀಡಿರುತ್ತಾರೆ.

ಈ ಕಾಮಗಾರಿಯನ್ನು ಕೈಗೊಳ್ಳಲು ತುಮಕೂರು ಸಣ್ಣ ನೀರಾವರಿ ವಿಭಾಗದಿಂದ ಕರೆಯಲಾದ ಟೆಂಡರ್ ಪ್ರಕಟಣೆಯನ್ನು ಕೆಳಕಂಡ ಮಾಧ್ಯಮಗಳಲ್ಲಿ ಪ್ರಕಟಿಸಲಾಗಿದೆ.

| | ಮೂಲ ಪ್ರಕಟಣೆ | ತಿದ್ದುಪಡಿ ಪ್ರಕಟಣೆ |
|---|---|---|
| ತುಮಕೂರು ಜಿಲ್ಲಾ ಟೆಂಡರ್ ಬುಲೆಟಿನ್ | 27-7-2012 | |
| ಪ್ರಜಾ ಪ್ರಗತಿ ದಿನ ಪತ್ರಿಕೆ | 29-7-2012 | 1-8-2012 |

ದಿನಾಂಕ 13-8-2012ರಂದು ಇ-ಪ್ರೊಕ್ಯೂರ್‌ಮೆಂಟ್ ಮೂಲಕ ಟೆಂಡರ್ ಅನ್ನು ತೆರೆಯಲಾಗಿದ್ದು, ಈ ಟೆಂಡರ್ ಪ್ರಕಟಣೆಗೆ ಸ್ಪಂದಿಸಿ ಇಬ್ಬರು ಗುತ್ತಿಗೆದಾರರು ಭಾಗವಹಿಸಿದ್ದು ಇವರಲ್ಲಿ ಒಬ್ಬರು ಟೆಂಡರ್ ಅರ್ಹತೆ ಹೊಂದಿದ್ದು, ವಿವರಗಳು ಕೆಳಕಂಡಂತಿವೆ.

| ಮಂಜೂರಾದ ಅಂದಾಜಿನ ದರಗಳಂತೆ ಹಾಗೂ ಪ್ರಸಕ್ತ ಸಾಲಿನ ದರಗಳಿಗೆ ಪರಿಷ್ಕರಿಸಿದಂತೆ ಟೆಂಡರಿಗೆ ಇಡಲಾದ ಮೊತ್ತ | | | ರೂ. 9,96,942/– |
|---|---|---|---|
| ಕ್ರಮ ಸಂಖ್ಯೆ | ಗುತ್ತಿಗೆದಾರರ ಹೆಸರು ಮತ್ತು ದರ್ಜೆ ಶ್ರೀ/ಮೆಸರ್ಸ್ | ಟೆಂಡರ್‌ನಲ್ಲಿ ಗುತ್ತಿಗೆದಾರರು ನಮೂದಿಸಿರುವ ದರಗಳಂತೆ ಟೆಂಡರಿನ ಮೊತ್ತ | ಮಂಜೂರಾದ ಅಂದಾಜಿನ ದರಗಳ ಹಾಗೂ ಪ್ರಸಕ್ತ ಸಾಲಿನ ದರಗಳ ಮೇಲಿನ ಶೇಕಡಾವಾರು ಹೆಚ್ಚಳ/ಕಡಿಮೆ |
| 1. | ರಾಮಚಂದ್ರ ರೆಡ್ಡಿ, 1ನೇ ದರ್ಜೆ ಗುತ್ತಿಗೆದಾರರು | 10,93,581/– | 9.69 ಹೆಚ್ಚು |

ಮೇಲ್ಕಂಡಂತೆ ಶ್ರೀ ರಾಮಚಂದ್ರ ರೆಡ್ಡಿ, 1ನೇ ದರ್ಜೆ ಗುತ್ತಿಗೆದಾರರು ಇವರು ಟೆಂಡರ್‌ನಲ್ಲಿ ಅರ್ಹತೆ ಹೊಂದಿದ ಗುತ್ತಿಗೆದಾರರಾಗಿದ್ದು ಇವರು ನಮೂದಿಸಿದ ದರಗಳನ್ನು ಪ್ರಸಕ್ತ ಸಾಲಿನ ದರಗಳಿಗೆ ಪರಿಷ್ಕರಿಸಿದ ಟೆಂಡರ್‌ಗಿಟ್ಟ ಮೊತ್ತಕ್ಕೆ ಹೋಲಿಸಿದಾಗ ಶೇಕಡ 9.69 ರಷ್ಟು ಹೆಚ್ಚಾಗಿರುತ್ತದೆ. ಸದರಿ ಟೆಂಡರನ್ನು ಸರ್ಕಾರದಲ್ಲಿ ಪರಿಶೀಲಿಸಿ ಪರಿಷ್ಕೃತ ದರಗಳ ಮೇಲೆ ಶೇ. 9.50ರಷ್ಟು ಹೆಚ್ಚಿನ ದರಗಳಿಗೆ ಅಂದರೆ ರೂ. 10,91,651/– ಗಳಿಗೆ ಟೆಂಡರನ್ನು ಅನುಮೋದಿಸಲು ಪರಿಗಣಿಸಿದೆ.

ಮೇಲಿನ ಅಂಶಗಳ ಹಿನ್ನೆಲೆಯಲ್ಲಿ ಸರ್ಕಾರವು ಈ ಕೆಳಕಂಡಂತೆ ಆದೇಶ ಹೊರಡಿಸಿದೆ.

**ಸರ್ಕಾರದ ಆದೇಶ ಸಂಖ್ಯೆ : ಸನೀಇ 65 ಕೆಜಿದು 2012 (ತಾಂತ್ರಿಕ), ಬೆಂಗಳೂರು, ದಿನಾಂಕ : 3ನೇ ಜನವರಿ, 2013.**

ಪ್ರಸ್ತಾವನೆಯಲ್ಲಿ ವಿವರಿಸಿರುವ ಅಂಶಗಳ ಹಿನ್ನೆಲೆಯಲ್ಲಿ ತುಮಕೂರು ಜಿಲ್ಲೆ, ಪಾವಗಡ ತಾಲ್ಲೂಕು, ತಿರುಮಣಿ ಕೆರೆ ಹೂಳೆತ್ತುವ ಕಾಮಗಾರಿಯನ್ನು ಪ್ರಸಕ್ತ ಸಾಲಿನ ದರಪಟ್ಟಿಯ ದರಗಳನ್ನು ಪರಿಗಣಿಸಿ ಪರಿಷ್ಕರಿಸಿದಂತೆ ಟೆಂಡರಿಗಿಟ್ಟ ಮೊತ್ತ ರೂ. 9,96,942/–ಗಳ ಮೇಲೆ ಶೇ. 9.50ರಷ್ಟು ಹೆಚ್ಚಿನ ದರದಲ್ಲಿ ಅಂದರೆ ರೂ. 10,91,651/–ಗಳಿಗೆ (ರೂ. ಹತ್ತು ಲಕ್ಷ ತೊಂಬತ್ತ ಒಂದು ಸಾವಿರದ ಆರು ನೂರ ಐವತ್ತ ಒಂದು ರೂಪಾಯಿಗಳು ಮಾತ್ರ) ಶ್ರೀ ರಾಮಚಂದ್ರ ರೆಡ್ಡಿ, 1ನೇ ದರ್ಜೆ ಗುತ್ತಿಗೆದಾರರಿಗೆ ಕೆಳಕಂಡ ಷರತ್ತುಗಳಿಗೆ ಒಳಪಡಿಸಿ ವಹಿಸಲು ಸರ್ಕಾರವು ಅನುಮೋದನೆ ನೀಡಿದೆ.

1. ಕಾಮಗಾರಿಯನ್ನು ನಿಗಧಿತ ಅವಧಿಯಲ್ಲಿ ಪೂರ್ಣಗೊಳಿಸತಕ್ಕದ್ದು.
2. ಸರ್ಕಾರದ ಅನುಮತಿ ಪಡೆಯದೆ ಕಾಮಗಾರಿಯಲ್ಲಿ ಯಾವುದೇ ಹೆಚ್ಚುವರಿ ಕೆಲಸ ನಿರ್ವಹಿಸಬಾರದು.

ಈ ಆದೇಶವನ್ನು ಆರ್ಥಿಕ ಇಲಾಖೆಯ ಆದೇಶ ಸಂಖ್ಯೆ : ಎಫ್‌ಡಿ 1 ಟಿಎಫ್‌ಪಿ 2002, ದಿನಾಂಕ : 20–1–2003 ರಲ್ಲಿ ಇಲಾಖಾ ಕಾರ್ಯದರ್ಶಿಯವರಿಗೆ ನೀಡಿರುವ ಆರ್ಥಿಕಾಧಿಕಾರದನ್ವಯ ಹೊರಡಿಸಲಾಗಿದೆ.

ಕರ್ನಾಟಕ ರಾಜ್ಯಪಾಲರ ಆದೇಶಾನುಸಾರ ಮತ್ತು ಅವರ ಹೆಸರಿನಲ್ಲಿ
**ರುದ್ರಮೂರ್ತಿ**
ಪದನಿಮಿತ್ತ ಸರ್ಕಾರದ ಅಧೀನ ಕಾರ್ಯದರ್ಶಿ,
ಜಲಸಂಪನ್ಮೂಲ ಇಲಾಖೆ (ಸಣ್ಣ ನೀರಾವರಿ).

P.R. 96

## ಜಲಸಂಪನ್ಮೂಲ ಸಚಿವಾಲಯ

**ವಿಷಯ :** ಹಾವೇರಿ ಜಿಲ್ಲೆ, ಹಾನಗಲ್ ತಾಲ್ಲೂಕಿನ ಆನಿ ಕೆರೆ ಸುಧಾರಣೆ ಕಾಮಗಾರಿಯ ಟೆಂಡರ್ ಅನುಮೋದಿಸುವ ಬಗ್ಗೆ.

**ಓದಲಾಗಿದೆ :**
1. ಸರ್ಕಾರದ ಆದೇಶ ಸಂಖ್ಯೆ : ಸನೀಇ 117 ಮಸಾವಿ 2011 (ತಾಂತ್ರಿಕ), ದಿನಾಂಕ : 22–2–2012
2. ಮುಖ್ಯ ಇಂಜಿನಿಯರ್, ಸಣ್ಣ ನೀರಾವರಿ ಉತ್ತರ ವಲಯ ಬಿಜಾಪುರರವರ ಪತ್ರದ ಸಂಖ್ಯೆ : ಮುಇಂ/ಸನೀ(ಉ) ವಲಯ/ಬಿಜೆಪಿ/ಎಇ–3/2012–13/5849, ದಿನಾಂಕ : 26–10–2012

**ಪ್ರಸ್ತಾವನೆ :**

ಹಾವೇರಿ ಜಿಲ್ಲೆ, ಹಾನಗಲ್ ತಾಲ್ಲೂಕಿನ ಆನಿ ಕೆರೆ ಸುಧಾರಣೆ ಕಾಮಗಾರಿ ಅಂದಾಜಿಗೆ ಉಲ್ಲೇಖ (1) ರಲ್ಲಿ ನಮೂದಿಸಿರುವ ಸರ್ಕಾರದ ಆದೇಶದಲ್ಲಿ ರೂ. 338.00 ಲಕ್ಷಗಳಿಗೆ ಆಡಳಿತಾತ್ಮಕ ಅನುಮೋದನೆ ನೀಡಲಾಗಿದ್ದು ಮುಖ್ಯ ಇಂಜಿನಿಯರ್, ಸಣ್ಣ ನೀರಾವರಿ ಉತ್ತರ ವಲಯ, ಬಿಜಾಪುರರವರು ತಾಂತ್ರಿಕ ಮಂಜೂರಾತಿ ನೀಡಿರುತ್ತಾರೆ.

ಈ ಕಾಮಗಾರಿಯನ್ನು ಕೈಗೊಳ್ಳಲು ಧಾರವಾಡ ಸಣ್ಣ ನೀರಾವರಿ ವಿಭಾಗದಿಂದ ಕರ್ನಾಟಕ ಸಾರ್ವಜನಿಕ ಸಂಗ್ರಹಣೆಗಳಲ್ಲಿ ಪಾರದರ್ಶಕತೆ ಅಧಿನಿಯಮದಡಿ ಇ–ಪ್ರೊಕ್ಯೂರ್‌ಮೆಂಟ್ ಮೂಲಕ ಕರೆಯಲಾದ ಟೆಂಡರ್ ಪ್ರಕಟಣೆಯನ್ನು ಕೆಳಕಂಡ ಮಾಧ್ಯಮಗಳಲ್ಲಿ ಪ್ರಕಟಿಸಲಾಗಿದೆ.

| | |
|---|---|
| ರಾಜ್ಯ ಟೆಂಡರ್ ಬುಲೆಟಿನ್ | 21–6–2012 |
| ಜಿಲ್ಲಾ ಟೆಂಡರ್ ಬುಲೆಟಿನ್ | 30–6–2012 |
| ವಿಜಯ ಕರ್ನಾಟಕ ದಿನ ಪತ್ರಿಕೆ | 25–6–2012 |
| ಸಂಯುಕ್ತ ಕರ್ನಾಟಕ ದಿನ ಪತ್ರಿಕೆ | 25–6–2012 |

ದಿನಾಂಕ : 29–8–2012 ರಂದು ಇ–ಪ್ರೊಕ್ಯೂರ್‌ಮೆಂಟ್ ಮೂಲಕ ಟೆಂಡರನ್ನು ತೆರೆದು ಪರಿಶೀಲಿಸಲಾಗಿರುತ್ತದೆ. ಈ ಟೆಂಡರ್ ಪ್ರಕಟಣೆಗೆ ಸ್ಪಂದಿಸಿ ಇಬ್ಬರು ಗುತ್ತಿಗೆದಾರರು ಭಾಗವಹಿಸಿದ್ದು ಈ ಪೈಕಿ ಒಬ್ಬರು ಗುತ್ತಿಗೆದಾರರು ಅರ್ಹತೆ ಹೊಂದಿರುತ್ತಾರೆ. ಇವರ ಆರ್ಥಿಕ ಬಿಡ್ ಅನ್ನು ದಿನಾಂಕ : 27–9–2012 ರಂದು ತೆರೆಯಲಾಗಿದ್ದು ವಿವರಗಳು ಕೆಳಕಂಡಂತಿವೆ.

| | | | |
|---|---|---|---|
| ಮಂಜೂರಾದ ಅಂದಾಜಿನ ದರಗಳಂತೆ ಟೆಂಡರಿಗೆ ಇಡಲಾದ ಮೊತ್ತ | | ರೂ. 3,30,19,488/– | |
| ಪ್ರಸಕ್ತ ಸಾಲಿನ ದರಗಳನ್ನು ಪರಿಗಣಿಸಿ ಪರಿಷ್ಕರಿಸಿದಂತೆ ಟೆಂಡರಿಗೆ ಇಡಲಾದ ಮೊತ್ತ | | ರೂ. 3,34,44,500/– | |
| ಗುತ್ತಿಗೆದಾರರ ಹೆಸರು ಮತ್ತು ದರ್ಜೆ ಶ್ರೀ/ಮೆಸರ್ಸ್ | ಟೆಂಡರ್‌ನಲ್ಲಿ ಗುತ್ತಿಗೆದಾರರು ನಮೂದಿಸಿರುವ ದರಗಳಂತೆ ಟೆಂಡರಿನ ಮೊತ್ತ | ಮಂಜೂರಾದ ಅಂದಾಜಿನ ದರಗಳ ಮೇಲಿನ ಶೇಕಡಾವಾರು ಹೆಚ್ಚಳ/ಕಡಿಮೆ | ಪರಿಷ್ಕರಿಸಿದ ದರಗಳ ಮೇಲಿನ ಶೇಕಡಾವಾರು ಹೆಚ್ಚಳ/ಕಡಿಮೆ |
| ವಿ.ಎಂ. ಹೆಬ್ಬಾಳ, 1ನೇ ದರ್ಜೆ ಗುತ್ತಿಗೆದಾರರು | 3,87,53,231/– | 17.36 ಹೆಚ್ಚು | 15.87 ಹೆಚ್ಚು |

ಮೇಲ್ಕಂಡಂತೆ ಶ್ರೀ ವಿ.ಎಂ. ಹೆಬ್ಬಾಳ, 1ನೇ ದರ್ಜೆ ಗುತ್ತಿಗೆದಾರರು ಇವರು ಟೆಂಡರ್‌ನಲ್ಲಿ ಅರ್ಹತೆ ಹೊಂದಿರುವ ಗುತ್ತಿಗೆದಾರರಾಗಿದ್ದು ಇವರು ನಮೂದಿಸಿದ ದರಗಳನ್ನು ಪ್ರಸಕ್ತ ಸಾಲಿನ ದರಗಳಿಗೆ ಪರಿಷ್ಕರಿಸಿದ ಟೆಂಡರ್‌ಗಿಟ್ಟ ಮೊತ್ತಕ್ಕೆ ಹೋಲಿಸಿದಾಗ ಶೇಕಡ 15.87 ರಷ್ಟು ಹೆಚ್ಚಾಗಿದ್ದು ಸದರಿಯವರ ಟೆಂಡರನ್ನು ಸಂಧಾನದ ಮೂಲಕ ಅಂಗೀಕರಿಸಲು ಮುಖ್ಯ ಇಂಜಿನಿಯರ್, ಸಣ್ಣ ನೀರಾವರಿ ಉತ್ತರ ವಲಯ, ಬಿಜಾಪುರ ಇವರು ಮೇಲೆ (2) ರಲ್ಲಿ ಓದಲಾದ ಪತ್ರದಲ್ಲಿ ಶಿಫಾರಸ್ಸು ಮಾಡಿರುತ್ತಾರೆ.

ಈ ಟೆಂಡರನ್ನು ಸರ್ಕಾರದಲ್ಲಿ ಪರಿಶೀಲಿಸಿ ಪ್ರಸಕ್ತ ಸಾಲಿನ ದರಗಳಿಗೆ ಪರಿಷ್ಕರಿಸಿದಂತೆ ಟೆಂಡರಿಗಿಟ್ಟ ಪರಿಷ್ಕೃತ ಮೊತ್ತ ರೂ. 3,34,44,500/–ಗಳ ಮೇಲೆ ಶೇಕಡಾ 13.00ರಷ್ಟು ಹೆಚ್ಚಿನ ದರಗಳಿಗೆ ಅಂದರೆ ರೂ. 3,77,92,285/– ಗಳಿಗೆ ಟೆಂಡರನ್ನು ಅನುಮೋದಿಸಲು ಪರಿಗಣಿಸಿದೆ.

ಮೇಲಿನ ಅಂಶಗಳ ಹಿನ್ನೆಲೆಯಲ್ಲಿ ಸರ್ಕಾರವು ಈ ಕೆಳಕಂಡಂತೆ ಆದೇಶ ಹೊರಡಿಸಿದೆ.

**ಸರ್ಕಾರದ ಆದೇಶ ಸಂಖ್ಯೆ : ಸನೀಇ 54 ಕೆಜಿದು (ತಾಂತ್ರಿಕ) 2012, ಬೆಂಗಳೂರು, ದಿನಾಂಕ : 23ನೇ ನವೆಂಬರ್, 2012.**

ಪ್ರಸ್ತಾವನೆಯಲ್ಲಿ ವಿವರಿಸಿರುವ ಅಂಶಗಳ ಹಿನ್ನೆಲೆಯಲ್ಲಿ ಹಾವೇರಿ ಜಿಲ್ಲೆ, ಹಾನಗಲ್ ತಾಲ್ಲೂಕಿನ ಆನಿ ಕೆರೆ ಸುಧಾರಣೆ ಕಾಮಗಾರಿಯನ್ನು ಪ್ರಸಕ್ತ ಸಾಲಿನ ದರಪಟ್ಟಿಯ ದರಗಳನ್ನು ಪರಿಗಣಿಸಿ ಪರಿಷ್ಕರಿಸಿದಂತೆ ಟೆಂಡರಿಗಿಡಲಾದ ಮೊತ್ತ ರೂ. 3,34,44,500/–ಗಳ ಮೇಲೆ ಶೇ. 13.00 ರಷ್ಟು ಹೆಚ್ಚಿನ ದರಗಳಿಗೆ ಅಂದರೆ ರೂ. 3,77,92,285/–ಗಳಿಗೆ (ರೂ. ಮೂರು ಕೋಟಿ ಎಪ್ಪತ್ತೇಳು ಲಕ್ಷ ತೊಂಬತ್ತೆರಡು ಸಾವಿರದ ಇನ್ನೂರ ಎಂಬತ್ತೈದು ಮಾತ್ರ) ಗಳಿಗೆ ಶ್ರೀ ವಿ.ಎಂ. ಹೆಬ್ಬಾಳ, ಒಂದನೇ ದರ್ಜೆ ಗುತ್ತಿಗೆದಾರರು ರವರಿಗೆ ಕೆಳಕಂಡ ಷರತ್ತುಗಳಿಗೆ ಒಳಪಡಿಸಿ ವಹಿಸಲು ಸರ್ಕಾರವು ಅನುಮೋದನೆ ನೀಡಿದೆ.

1. ಕಾಮಗಾರಿಯನ್ನು ನಿಗಧಿತ ಅವಧಿಯಲ್ಲಿ ಪೂರ್ಣಗೊಳಿಸತಕ್ಕದ್ದು.
2. ಸರ್ಕಾರದ ಅನುಮತಿ ಪಡೆಯದೆ ಕಾಮಗಾರಿಯಲ್ಲಿ ಯಾವುದೇ ಹೆಚ್ಚುವರಿ ಕೆಲಸ ನಿರ್ವಹಿಸಬಾರದು.

ಈ ಆದೇಶವನ್ನು ಆರ್ಥಿಕ ಇಲಾಖೆಯ ಆದೇಶ ಸಂಖ್ಯೆ : ಎಫ್‌ಡಿ 1 ಟಿಎಫ್‌ಪಿ 2002, ದಿನಾಂಕ : 20–1–2003 ರಲ್ಲಿ ಇಲಾಖಾ ಕಾರ್ಯದರ್ಶಿಯವರಿಗೆ ನೀಡಿರುವ ಆರ್ಥಿಕಾಧಿಕಾರದನ್ವಯ ಹೊರಡಿಸಲಾಗಿದೆ.

ಕರ್ನಾಟಕ ರಾಜ್ಯಪಾಲರ ಆದೇಶಾನುಸಾರ ಮತ್ತು ಅವರ ಹೆಸರಿನಲ್ಲಿ

**ರುದ್ರಮೂರ್ತಿ**

ಪದನಿಮಿತ್ತ ಸರ್ಕಾರದ ಅಧೀನ ಕಾರ್ಯದರ್ಶಿ,

ಜಲಸಂಪನ್ಮೂಲ ಇಲಾಖೆ (ಸಣ್ಣ ನೀರಾವರಿ).

**P.R. 2221**

## ಜಲಸಂಪನ್ಮೂಲ ಸಚಿವಾಲಯ

**ವಿಷಯ :** ಬಾಗಲಕೋಟೆ ಜಿಲ್ಲೆ ಬದಾಮಿ ತಾಲ್ಲೂಕಿನ ಹೂವಿನಹಳ್ಳಿ ಏತ ನೀರಾವರಿ ಯೋಜನೆಯ ಸುಧಾರಣೆ (ಎಕ್ಸ್‌ಪ್ರೆಸ್ ಫೀಡರ್ ಲೈನ್) ಕಾಮಗಾರಿಗಳ ಟೆಂಡರ್ ಅನುಮೋದಿಸುವ ಬಗ್ಗೆ.

**ಓದಲಾಗಿದೆ :**

1. ಸರ್ಕಾರದ ಆದೇಶ ಸಂಖ್ಯೆ : ಸನೀಇ 03 ನಯೋಕಾ 2011, ದಿನಾಂಕ : 22–2–2012
2. ಮುಖ್ಯ ಇಂಜಿನಿಯರ್, ಸಣ್ಣ ನೀರಾವರಿ ಉತ್ತರ ವಲಯ ಬಿಜಾಪುರರವರ ಪತ್ರದ ಸಂಖ್ಯೆ : ಮುಇಂ/ಸನೀ(ಉ)ವಲಯ/ಬಿಜೆಪಿ/ಎಇ–6/2012–13/6509, ದಿನಾಂಕ : 30–11–2012

**ಪ್ರಸ್ತಾವನೆ :**

ಬಾಗಲಕೋಟೆ ಜಿಲ್ಲೆ ಬದಾಮಿ ತಾಲ್ಲೂಕಿನ ಹೂವಿನಹಳ್ಳಿ ಏತ ನೀರಾವರಿ ಯೋಜನೆಯ ಸುಧಾರಣೆ (ಎಕ್ಸ್‌ಪ್ರೆಸ್ ಫೀಡರ್ ಲೈನ್) ಕಾಮಗಾರಿಯ ಅಂದಾಜಿಗೆ ಉಲ್ಲೇಖ (1) ರಲ್ಲಿ ನಮೂದಿಸಿರುವ ಸರ್ಕಾರದ ಆದೇಶದಲ್ಲಿ ರೂ. 30.50 ಲಕ್ಷಗಳಿಗೆ ನಬಾರ್ಡ್‌ನ ಆರ್.ಐ.ಡಿ.ಎಫ್–17 ಯೋಜನೆಯಡಿ ಆಡಳಿತಾತ್ಮಕ ಅನುಮೋದನೆ ನೀಡಲಾಗಿದ್ದು ಮುಖ್ಯ ಇಂಜಿನಿಯರ್, ಸಣ್ಣ ನೀರಾವರಿ ಉತ್ತರ ವಲಯ, ಬಿಜಾಪುರರವರು ತಾಂತ್ರಿಕ ಮಂಜೂರಾತಿ ನೀಡಿರುತ್ತಾರೆ.

ಈ ಕಾಮಗಾರಿಯನ್ನು ಕೈಗೊಳ್ಳಲು ಬಿಜಾಪುರ ಸಣ್ಣ ನೀರಾವರಿ ವಿಭಾಗದಿಂದ ಕರ್ನಾಟಕ ಸಾರ್ವಜನಿಕ ಸಂಗ್ರಹಣೆಗಳಲ್ಲಿ ಪಾರದರ್ಶಕತೆ ಅಧಿನಿಯಮದಡಿ ಇ–ಪ್ರೊಕ್ಯೂರ್‌ಮೆಂಟ್ ಮೂಲಕ ಕರೆಯಲಾದ ಟೆಂಡರ್ ಪ್ರಕಟಣೆಯನ್ನು ಕೆಳಕಂಡ ಮಾಧ್ಯಮಗಳಲ್ಲಿ ಪ್ರಕಟಿಸಲಾಗಿದೆ.

| | |
|---|---|
| ಜಿಲ್ಲಾ ಟೆಂಡರ್ ಬುಲೆಟಿನ್ | 29–9–2012 |
| ಕನ್ನಡ ಪ್ರಭ ಬುಲೆಟಿನ್ | 26–9–2012 |

ದಿನಾಂಕ : 12–10–2012 ರಂದು ಇ–ಪ್ರೊಕ್ಯೂರ್‌ಮೆಂಟ್ ಮೂಲಕ ಟೆಂಡರನ್ನು ತೆರೆದು ಪರಿಶೀಲಿಸಲಾಗಿರುತ್ತದೆ. ಈ ಟೆಂಡರ್ ಪ್ರಕಟಣೆಗೆ ಸ್ಪಂದಿಸಿ ಇಬ್ಬರು ಗುತ್ತಿಗೆದಾರರು ಭಾಗವಹಿಸಿದ್ದು ಇವರು ಅರ್ಹತೆ ಹೊಂದಿರುತ್ತಾರೆ. ವಿವರಗಳು ಕೆಳಕಂಡಂತಿವೆ.

| | | | |
|---|---|---|---|
| ಮಂಜೂರಾದ ಅಂದಾಜಿನ ದರಗಳಂತೆ ಟೆಂಡರಿಗೆ ಇಡಲಾದ ಮೊತ್ತ | | | ರೂ. 24,36,302/– |
| ಪ್ರಸಕ್ತ ಸಾಲಿನ ದರಗಳನ್ನು ಪರಿಗಣಿಸಿ ಪರಿಷ್ಕರಿಸಿದಂತೆ ಟೆಂಡರಿಗೆ ಇಡಲಾದ ಮೊತ್ತ | | | ರೂ. 32,57,683/– |
| ಗುತ್ತಿಗೆದಾರರ ಹೆಸರು ಮತ್ತು ದರ್ಜೆ ಶ್ರೀ/ಮೆಸರ್ಸ್ | ಟೆಂಡರ್‌ನಲ್ಲಿ ಗುತ್ತಿಗೆದಾರರು ನಮೂದಿಸಿರುವ ದರಗಳಂತೆ ಟೆಂಡರಿನ ಮೊತ್ತ | ಮಂಜೂರಾದ ಅಂದಾಜಿನ ದರಗಳ ಮೇಲಿನ ಶೇಕಡಾವಾರು ಹೆಚ್ಚಳ/ಕಡಿಮೆ | ಪರಿಷ್ಕರಿಸಿದ ದರಗಳ ಮೇಲಿನ ಶೇಕಡಾವಾರು ಹೆಚ್ಚಳ/ಕಡಿಮೆ |
| ಅಶೋಕ ಶೆಟ್ಟಿ, 1ನೇ ದರ್ಜೆ ಗುತ್ತಿಗೆದಾರರು | 35,97,513 /– | 47.66 ಹೆಚ್ಚು | 10.43 ಹೆಚ್ಚು |
| ಆರ್.ಎಸ್. ಹಳ್ಳದ (ಗುರುದತ್ತ ಎಲೆಕ್ಟ್ರಿಕಲ್ಸ್) ಗುತ್ತಿಗೆದಾರರು | 41,19,100/– | 69.07 ಹೆಚ್ಚು | 26.44 ಹೆಚ್ಚು |

ಮೇಲ್ಕಂಡಂತೆ ಶ್ರೀ ಅಶೋಕ ಎಸ್. ಶೆಟ್ಟಿ, 1ನೇ ದರ್ಜೆ ಗುತ್ತಿಗೆದಾರರು ಇವರು ಟೆಂಡರ್‌ನಲ್ಲಿ ಅರ್ಹತೆ ಹೊಂದಿರುವ ಗುತ್ತಿಗೆದಾರರಾಗಿದ್ದು ಇವರು ನಮೂದಿಸಿದ ದರಗಳನ್ನು ಪ್ರಸಕ್ತ ಸಾಲಿನ ದರಗಳಿಗೆ ಪರಿಷ್ಕರಿಸಿದ ಟೆಂಡರ್‌ಗಿಟ್ಟ ಮೊತ್ತಕ್ಕೆ ಹೋಲಿಸಿದಾಗ ಶೇಕಡ 10.43ರಷ್ಟು ಹೆಚ್ಚಾಗಿದ್ದು, ಸದರಿಯವರ ಟೆಂಡರನ್ನು ಸಂದಾನದ ಮೂಲಕ ಅಂಗೀಕರಿಸಲು ಮುಖ್ಯ ಇಂಜಿನಿಯರ್, ಸಣ್ಣ ನೀರಾವರಿ ಉತ್ತರ ವಲಯ, ಬಿಜಾಪುರ ಇವರು ಮೇಲೆ (2) ರಲ್ಲಿ ಓದಲಾದ ಪತ್ರದಲ್ಲಿ ಶಿಫಾರಸ್ಸು ಮಾಡಿರುತ್ತಾರೆ.

ಈ ಟೆಂಡರನ್ನು ಸರ್ಕಾರದಲ್ಲಿ ಪರಿಶೀಲಿಸಿ ಪ್ರಸಕ್ತ ಸಾಲಿನ ದರಗಳಿಗೆ ಪರಿಷ್ಕರಿಸಿದಂತೆ ಟೆಂಡರಿಗಿಟ್ಟ ಪರಿಷ್ಕೃತ ಮೊತ್ತ ರೂ. 32,57,683/–ಗಳ ಮೇಲೆ ಶೇಕಡಾ 10.25ರಷ್ಟು ಹೆಚ್ಚಿನ ದರಗಳಿಗೆ ಅಂದರೆ ರೂ. 35,91,569/– ಗಳಿಗೆ ಟೆಂಡರನ್ನು ಅನುಮೋದಿಸಲು ಪರಿಗಣಿಸಿದೆ.

ಮೇಲಿನ ಅಂಶಗಳ ಹಿನ್ನೆಲೆಯಲ್ಲಿ ಸರ್ಕಾರವು ಈ ಕೆಳಕಂಡಂತೆ ಆದೇಶ ಹೊರಡಿಸಿದೆ.

**ಸರ್ಕಾರದ ಆದೇಶ ಸಂಖ್ಯೆ : ಸನೀಇ 04 ಏನೀಯೋ (ತಾಂತ್ರಿಕ) 2013, ಬೆಂಗಳೂರು, ದಿನಾಂಕ : 17ನೇ ಜನವರಿ, 2013.**

ಪ್ರಸ್ತಾವನೆಯಲ್ಲಿ ವಿವರಿಸಿರುವ ಅಂಶಗಳ ಹಿನ್ನೆಲೆಯಲ್ಲಿ ಬಾಗಲಕೋಟೆ ಜಿಲ್ಲೆ ಬದಾಮಿ ತಾಲ್ಲೂಕಿನ ಹೂವಿನಹಳ್ಳಿ ಏತ ನೀರಾವರಿ ಯೋಜನೆಯ ಸುಧಾರಣೆ (ಎಕ್ಸ್‌ಪ್ರೆಸ್ ಫೀಡರ್ ಲೈನ್) ಕಾಮಗಾರಿಯನ್ನು ಪ್ರಸಕ್ತ ಸಾಲಿನ ದರಪಟ್ಟಿಯ ದರಗಳನ್ನು ಪರಿಗಣಿಸಿ ಪರಿಷ್ಕರಿಸಿದಂತೆ ಟೆಂಡರಿಗಿಡಲಾದ ಮೊತ್ತ ರೂ. 32,57,683/–ಗಳ ಮೇಲೆ ಶೇ. 10.25 ರಷ್ಟು ಹೆಚ್ಚಿನ ದರಗಳಿಗೆ ಅಂದರೆ ರೂ. 35,91,596/–ಗಳಿಗೆ (ರೂ. ಮೂವತ್ತೈದು ಲಕ್ಷ ತೊಂಬತ್ತೊಂದು ಸಾವಿರದ ಐನೂರ ತೊಂಬತ್ತಾರು ಮಾತ್ರ) ಗಳಿಗೆ ಶ್ರೀ ಅಶೋಕ ಶೆಟ್ಟಿ, ಒಂದನೇ ದರ್ಜೆ ಗುತ್ತಿಗೆದಾರ ರವರಿಗೆ ಕೆಳಕಂಡ ಷರತ್ತುಗಳಿಗೆ ಒಳಪಡಿಸಿ ವಹಿಸಲು ಸರ್ಕಾರವು ಅನುಮೋದನೆ ನೀಡಿದೆ.

1. ಕಾಮಗಾರಿಯನ್ನು ನಿಗಧಿತ ಅವಧಿಯಲ್ಲಿ ಪೂರ್ಣಗೊಳಿಸತಕ್ಕದ್ದು.
2. ಸರ್ಕಾರದ ಅನುಮತಿ ಪಡೆಯದೆ ಕಾಮಗಾರಿಯಲ್ಲಿ ಯಾವುದೇ ಹೆಚ್ಚುವರಿ ಕೆಲಸ ನಿರ್ವಹಿಸಬಾರದು.

ಈ ಆದೇಶವನ್ನು ಆರ್ಥಿಕ ಇಲಾಖೆಯ ಆದೇಶ ಸಂಖ್ಯೆ : ಎಫ್‌ಡಿ 1 ಟಿಎಫ್‌ಪಿ 2002, ದಿನಾಂಕ : 20–1–2003 ರಲ್ಲಿ ಇಲಾಖಾ ಕಾರ್ಯದರ್ಶಿಯವರಿಗೆ ನೀಡಿರುವ ಆರ್ಥಿಕಾಧಿಕಾರದನ್ವಯ ಹೊರಡಿಸಲಾಗಿದೆ.

ಕರ್ನಾಟಕ ರಾಜ್ಯಪಾಲರ ಆದೇಶಾನುಸಾರ ಮತ್ತು ಅವರ ಹೆಸರಿನಲ್ಲಿ
**ರುದ್ರಮೂರ್ತಿ**
ಪದನಿಮಿತ್ತ ಸರ್ಕಾರದ ಅಧೀನ ಕಾರ್ಯದರ್ಶಿ,
ಜಲಸಂಪನ್ಮೂಲ ಇಲಾಖೆ (ಸಣ್ಣ ನೀರಾವರಿ).

**P.R. 115**

## ಜಲಸಂಪನ್ಮೂಲ ಸಚಿವಾಲಯ

**ವಿಷಯ :** ಬಾಗಲಕೋಟೆ ಜಿಲ್ಲೆ ಬದಾಮಿ ತಾಲ್ಲೂಕಿನ ಆಲೂರ ಏತ ನೀರಾವರಿ ಯೋಜನೆಯ ಸುಧಾರಣೆ (ಎಕ್ಸ್‌ಪ್ರೆಸ್ ಫೀಡರ್ ಲೈನ್) ಕಾಮಗಾರಿಯ ಟೆಂಡರ್ ಅನುಮೋದಿಸುವ ಬಗ್ಗೆ.

**ಓದಲಾಗಿದೆ :**
1. ಸರ್ಕಾರದ ಆದೇಶ ಸಂಖ್ಯೆ : ಸನೀಇ 03 ನಯೋಕಾ 2011, ದಿನಾಂಕ : 13–2–2012
2. ಮುಖ್ಯ ಇಂಜಿನಿಯರ್, ಸಣ್ಣ ನೀರಾವರಿ ಉತ್ತರ ವಲಯ ಬಿಜಾಪುರರವರ ಪತ್ರದ ಸಂಖ್ಯೆ : ಮುಇಂ/ಸನೀ(ಉ)ವಲಯ/ಬಿಜೆಪಿ/ಎಇ–6/2012–13/6508, ದಿನಾಂಕ : 30–11–2012

**ಪ್ರಸ್ತಾವನೆ :**

ಬಾಗಲಕೋಟೆ ಜಿಲ್ಲೆ ಬದಾಮಿ ತಾಲ್ಲೂಕಿನ ಆಲೂರ ಏತ ನೀರಾವರಿ ಯೋಜನೆಯ ಸುಧಾರಣೆ (ಎಕ್ಸ್‌ಪ್ರೆಸ್ ಫೀಡರ್ ಲೈನ್) ಕಾಮಗಾರಿಯ ಅಂದಾಜಿಗೆ ಉಲ್ಲೇಖ (1) ರಲ್ಲಿ ನಮೂದಿಸಿರುವ ಸರ್ಕಾರದ ಆದೇಶದಲ್ಲಿ ರೂ. 30.00 ಲಕ್ಷಗಳಿಗೆ ನಬಾರ್ಡ್‌ನ ಆರ್.ಐ.ಡಿ.ಎಫ್–17 ಯೋಜನೆಯಡಿ ಆಡಳಿತಾತ್ಮಕ ಅನುಮೋದನೆ ನೀಡಲಾಗಿದ್ದು ಮುಖ್ಯ ಇಂಜಿನಿಯರ್, ಸಣ್ಣ ನೀರಾವರಿ ಉತ್ತರ ವಲಯ, ಬಿಜಾಪುರರವರು ತಾಂತ್ರಿಕ ಮಂಜೂರಾತಿ ನೀಡಿರುತ್ತಾರೆ.

ಈ ಕಾಮಗಾರಿಯನ್ನು ಕೈಗೊಳ್ಳಲು ಬಿಜಾಪುರ ಸಣ್ಣ ನೀರಾವರಿ ವಿಭಾಗದಿಂದ ಕರ್ನಾಟಕ ಸಾರ್ವಜನಿಕ ಸಂಗ್ರಹಣೆಗಳಲ್ಲಿ ಪಾರದರ್ಶಕತೆ ಅಧಿನಿಯಮದಡಿ ಇ–ಪ್ರೊಕ್ಯೂರ್‌ಮೆಂಟ್ ಮೂಲಕ ಕರೆಯಲಾದ ಟೆಂಡರ್ ಪ್ರಕಟಣೆಯನ್ನು ಕೆಳಕಂಡ ಮಾಧ್ಯಮಗಳಲ್ಲಿ ಪ್ರಕಟಿಸಲಾಗಿದೆ.

| | |
|---|---|
| ಜಿಲ್ಲಾ ಟೆಂಡರ್ ಬುಲೆಟಿನ್ | 29–9–2012 |
| ಕನ್ನಡ ಪ್ರಭ ಬುಲೆಟಿನ್ | 26–9–2012 |

ದಿನಾಂಕ : 12–10–2012 ರಂದು ಇ–ಪ್ರೊಕ್ಯೂರ್‌ಮೆಂಟ್ ಮೂಲಕ ಟೆಂಡರನ್ನು ತೆರೆದು ಪರಿಶೀಲಿಸಲಾಗಿರುತ್ತದೆ. ಈ ಟೆಂಡರ್ ಪ್ರಕಟಣೆಗೆ ಸ್ಪಂದಿಸಿ ಇಬ್ಬರು ಗುತ್ತಿಗೆದಾರರು ಭಾಗವಹಿಸಿದ್ದು ಇವರು ಅರ್ಹತೆ ಹೊಂದಿರುತ್ತಾರೆ. ವಿವರಗಳು ಕೆಳಕಂಡಂತಿವೆ.

| | | | |
|---|---|---|---|
| ಮಂಜೂರಾದ ಅಂದಾಜಿನ ದರಗಳಂತೆ ಟೆಂಡರಿಗೆ ಇಡಲಾದ ಮೊತ್ತ | | | ರೂ. 19,70,778/– |
| ಪ್ರಸಕ್ತ ಸಾಲಿನ ದರಗಳನ್ನು ಪರಿಗಣಿಸಿ ಪರಿಷ್ಕರಿಸಿದಂತೆ ಟೆಂಡರಿಗೆ ಇಡಲಾದ ಮೊತ್ತ | | | ರೂ. 23,65,828/– |
| ಗುತ್ತಿಗೆದಾರರ ಹೆಸರು ಮತ್ತು ದರ್ಜೆ ಶ್ರೀ/ಮೆಸರ್ಸ್ | ಟೆಂಡರ್‌ನಲ್ಲಿ ಗುತ್ತಿಗೆದಾರರು ನಮೂದಿಸಿರುವ ದರಗಳಂತೆ ಟೆಂಡರಿನ ಮೊತ್ತ | ಮಂಜೂರಾದ ಅಂದಾಜಿನ ದರಗಳ ಮೇಲಿನ ಶೇಕಡಾವಾರು ಹೆಚ್ಚಳ/ಕಡಿಮೆ | ಪರಿಷ್ಕರಿಸಿದ ದರಗಳ ಮೇಲಿನ ಶೇಕಡಾವಾರು ಹೆಚ್ಚಳ/ಕಡಿಮೆ |
| ಆರ್.ಎಸ್. ಹಳ್ಳದ, (ಗುರುದತ್ತ ಎಲೆಕ್ಟ್ರಿಕಲ್ಸ್) ಗುತ್ತಿಗೆದಾರರು | 28,28,300/– | 43.51 ಹೆಚ್ಚು | 19.55 ಹೆಚ್ಚು |
| ಅಶೋಕ ಶೆಟ್ಟಿ, 1ನೇ ದರ್ಜೆ ಗುತ್ತಿಗೆದಾರರು | 30,11,080/– | 52.78 ಹೆಚ್ಚು | 27.27 ಹೆಚ್ಚು |

ಮೇಲ್ಕಂಡಂತೆ ಶ್ರೀ ಆರ್.ಎಸ್. ಹಳ್ಳದ, 1ನೇ ದರ್ಜೆ ಗುತ್ತಿಗೆದಾರರು ಇವರು ಟೆಂಡರ್‌ನಲ್ಲಿ ಅರ್ಹತೆ ಹೊಂದಿದ ಗುತ್ತಿಗೆದಾರರಾಗಿದ್ದು ಇವರು ನಮೂದಿಸಿದ ದರಗಳನ್ನು ಪ್ರಸಕ್ತ ಸಾಲಿನ ದರಗಳಿಗೆ ಪರಿಷ್ಕರಿಸಿದಂತೆ ಟೆಂಡರ್‌ಗಿಟ್ಟ ಮೊತ್ತಕ್ಕೆ ಹೋಲಿಸಿದಾಗ ಶೇಕಡ 19.55ರಷ್ಟು ಹೆಚ್ಚಾಗಿದ್ದು, ಸದರಿಯವರ ಟೆಂಡರನ್ನು ಸಂಧಾನದ ಮೂಲಕ ಅಂಗೀಕರಿಸಲು ಮುಖ್ಯ ಇಂಜಿನಿಯರ್, ಸಣ್ಣ ನೀರಾವರಿ ಉತ್ತರ ವಲಯ, ಬಿಜಾಪುರ ಇವರು ಮೇಲೆ (2) ರಲ್ಲಿ ಓದಲಾದ ಪತ್ರದಲ್ಲಿ ಶಿಫಾರಸ್ಸು ಮಾಡಿರುತ್ತಾರೆ.

ಈ ಟೆಂಡರನ್ನು ಸರ್ಕಾರದಲ್ಲಿ ಪರಿಶೀಲಿಸಿ ಪ್ರಸಕ್ತ ಸಾಲಿನ ದರಗಳಿಗೆ ಪರಿಷ್ಕರಿಸಿದಂತೆ ಟೆಂಡರಿಗಿಟ್ಟ ಪರಿಷ್ಕೃತ ಮೊತ್ತ ರೂ. 23,65,828/– ಗಳ ಮೇಲೆ ಶೇಕಡಾ 14.90 ರಷ್ಟು ಹೆಚ್ಚಿನ ದರಗಳಿಗೆ ಅಂದರೆ ರೂ. 27,18,336/–ಗಳಿಗೆ ಟೆಂಡರನ್ನು ಅನುಮೋದಿಸಲು ಪರಿಗಣಿಸಿದೆ.

ಮೇಲಿನ ಅಂಶಗಳ ಹಿನ್ನೆಲೆಯಲ್ಲಿ ಸರ್ಕಾರವು ಈ ಕೆಳಕಂಡಂತೆ ಆದೇಶ ಹೊರಡಿಸಿದೆ.

**ಸರ್ಕಾರದ ಆದೇಶ ಸಂಖ್ಯೆ : ಸನೀಇ 05 ಏನೀಯೋ (ತಾಂತ್ರಿಕ) 2013, ಬೆಂಗಳೂರು, ದಿನಾಂಕ : 17ನೇ ಜನವರಿ, 2013.**

ಪ್ರಸ್ತಾವನೆಯಲ್ಲಿ ವಿವರಿಸಿರುವ ಅಂಶಗಳ ಹಿನ್ನೆಲೆಯಲ್ಲಿ ಬಾಗಲಕೋಟೆ ಜಿಲ್ಲೆ ಬದಾಮಿ ತಾಲ್ಲೂಕಿನ ಆಲೂರ ಏತ ನೀರಾವರಿ ಯೋಜನೆಯ ಸುಧಾರಣೆ (ಎಕ್ಸ್‌ಪ್ರೆಸ್ ಫೀಡರ್ ಲೈನ್) ಕಾಮಗಾರಿಯನ್ನು ಪ್ರಸಕ್ತ ಸಾಲಿನ ದರಪಟ್ಟಿಯ ದರಗಳನ್ನು ಪರಿಗಣಿಸಿ ಪರಿಷ್ಕರಿಸಿದಂತೆ ಟೆಂಡರಿಗಿಡಲಾದ ಮೊತ್ತ ರೂ. 23,65,828/–ಗಳ ಮೇಲೆ ಶೇ. 14.90ರಷ್ಟು ಹೆಚ್ಚಿನ ದರಗಳಿಗೆ ಅಂದರೆ ರೂ. 27,18,336/–ಗಳಿಗೆ (ರೂ. ಇಪ್ಪತ್ತೇಳು ಲಕ್ಷ ಹದಿನೆಂಟು ಸಾವಿರದ ಮುನ್ನೂರ ಮೂವತ್ತಾರು ಮಾತ್ರ) ಗಳಿಗೆ ಶ್ರೀ ಆರ್.ಎಸ್. ಹಳ್ಳದ, ಒಂದನೇ ದರ್ಜೆ ಗುತ್ತಿಗೆದಾರ ರವರಿಗೆ ಕೆಳಕಂಡ ಷರತ್ತುಗಳಿಗೆ ಒಳಪಡಿಸಿ ವಹಿಸಲು ಸರ್ಕಾರವು ಅನುಮೋದನೆ ನೀಡಿದೆ.

1. ಕಾಮಗಾರಿಯನ್ನು ನಿಗಧಿತ ಅವಧಿಯಲ್ಲಿ ಪೂರ್ಣಗೊಳಿಸತಕ್ಕದ್ದು.
2. ಸರ್ಕಾರದ ಅನುಮತಿ ಪಡೆಯದೆ ಕಾಮಗಾರಿಯಲ್ಲಿ ಯಾವುದೇ ಹೆಚ್ಚುವರಿ ಕೆಲಸ ನಿರ್ವಹಿಸಬಾರದು.

ಈ ಆದೇಶವನ್ನು ಆರ್ಥಿಕ ಇಲಾಖೆಯ ಆದೇಶ ಸಂಖ್ಯೆ : ಎಫ್‌ಡಿ 1 ಟಿಎಫ್‌ಪಿ 2002, ದಿನಾಂಕ : 20–1–2003ರಲ್ಲಿ ಇಲಾಖಾ ಕಾರ್ಯದರ್ಶಿಯವರಿಗೆ ನೀಡಿರುವ ಆರ್ಥಿಕಾಧಿಕಾರದನ್ವಯ ಹೊರಡಿಸಲಾಗಿದೆ.

ಕರ್ನಾಟಕ ರಾಜ್ಯಪಾಲರ ಆದೇಶಾನುಸಾರ ಮತ್ತು ಅವರ ಹೆಸರಿನಲ್ಲಿ
**ರುದ್ರಮೂರ್ತಿ**
ಪದನಿಮಿತ್ತ ಸರ್ಕಾರದ ಅಧೀನ ಕಾರ್ಯದರ್ಶಿ,
ಜಲಸಂಪನ್ಮೂಲ ಇಲಾಖೆ (ಸಣ್ಣ ನೀರಾವರಿ).

P.R. 121

## ಜಲಸಂಪನ್ಮೂಲ ಸಚಿವಾಲಯ

**ವಿಷಯ :** ಬೆಳಗಾವಿ ಜಿಲ್ಲೆ ಚಿಕ್ಕೋಡಿ ತಾಲ್ಲೂಕಿನ ಅಕ್ಕೋಳ ಗ್ರಾಮದ ಹತ್ತಿರ ವೇದಗಂಗಾ ನದಿಯಿಂದ ಏತ ನೀರಾವರಿ ಯೋಜನೆ ನಿರ್ಮಾಣ ಕಾಮಗಾರಿಯ ಟೆಂಡರ್ ಅನುಮೋದಿಸುವ ಬಗ್ಗೆ.

**ಓದಲಾಗಿದೆ :** ಮುಖ್ಯ ಇಂಜಿನಿಯರ್, ಸಣ್ಣ ನೀರಾವರಿ ಉತ್ತರ ವಲಯ ಬಿಜಾಪುರರವರ ಪತ್ರದ ಸಂಖ್ಯೆ : ಮುಇಂ/ಸನೀ(ಉ)ವಲಯ/ಬಿಜೆಪಿ/ಎಇ–1/2012–13/6202, ದಿನಾಂಕ : 17–11–2012

**ಪ್ರಸ್ತಾವನೆ :**

2012–13ನೇ ಸಾಲಿನ ವಿಶೇಷ ಘಟಕ ಯೋಜನೆ ಕಾರ್ಯಕ್ರಮದಡಿ ಅನುಮೋದನೆಗೊಂಡಿರುವ ಬೆಳಗಾವಿ ಜಿಲ್ಲೆ ಚಿಕ್ಕೋಡಿ ತಾಲ್ಲೂಕಿನ ಅಕ್ಕೋಳ ಗ್ರಾಮದ ಹತ್ತಿರ ವೇದಗಂಗಾ ನದಿಯಿಂದ ಏತ ನೀರಾವರಿ ಯೋಜನೆ ನಿರ್ಮಾಣ ಕಾಮಗಾರಿಯ ರೂ. 10.00 ಲಕ್ಷಗಳ ಅಂದಾಜು ಪಟ್ಟಿಗೆ ಕಾರ್ಯಪಾಲಕ ಅಭಿಯಂತರರು, ಸಣ್ಣ ನೀರಾವರಿ ವಿಭಾಗ, ಬೆಳಗಾವಿರವರು ಆಡಳಿತಾತ್ಮಕ ಅನುಮೋದನೆ ಹಾಗೂ ತಾಂತ್ರಿಕ ಮಂಜೂರಾತಿ ನೀಡಿರುತ್ತಾರೆ.

ಈ ಕಾಮಗಾರಿಯನ್ನು ಕೈಗೊಳ್ಳಲು ಬೆಳಗಾವಿ ಸಣ್ಣ ನೀರಾವರಿ ವಿಭಾಗದಿಂದ ಕರ್ನಾಟಕ ಸಾರ್ವಜನಿಕ ಸಂಗ್ರಹಣೆಗಳಲ್ಲಿ ಪಾರದರ್ಶಕತೆ ಅಧಿನಿಯಮದಡಿ ಇ–ಪ್ರೊಕ್ಯೂರ್‌ಮೆಂಟ್ ಮೂಲಕ ಕರೆಯಲಾದ ಟೆಂಡರ್ ಪ್ರಕಟಣೆಯನ್ನು ಕೆಳಕಂಡ ಮಾಧ್ಯಮಗಳಲ್ಲಿ ಪ್ರಕಟಿಸಲಾಗಿದೆ.

| | |
|---|---|
| ಜಿಲ್ಲಾ ಟೆಂಡರ್ ಬುಲೆಟಿನ್ | ದಿನಾಂಕ : 16–10–2012 |

ದಿನಾಂಕ : 22–10–2012 ರಂದು ಇ–ಪ್ರೊಕ್ಯೂರ್‌ಮೆಂಟ್ ಮೂಲಕ ಟೆಂಡರನ್ನು ತೆರೆದು ಪರಿಶೀಲಿಸಲಾಗಿರುತ್ತದೆ. ಈ ಟೆಂಡರ್ ಪ್ರಕಟಣೆಗೆ ಸ್ಪಂದಿಸಿ ಒಬ್ಬರು ಗುತ್ತಿಗೆದಾರರು ಭಾಗವಹಿಸಿದ್ದು ಇವರು ಅರ್ಹತೆ ಹೊಂದಿರುತ್ತಾರೆ. ವಿವರಗಳು ಕೆಳಕಂಡಂತಿವೆ.

| | | |
|---|---|---|
| ಮಂಜೂರಾದ ಅಂದಾಜಿನ ದರಗಳಂತೆ ಹಾಗೂ ಪ್ರಸಕ್ತ ಸಾಲಿನ ದರಗಳನ್ನು ಪರಿಗಣಿಸಿ ಪರಿಷ್ಕರಿಸಿದಂತೆ ಟೆಂಡರಿಗೆ ಇಡಲಾದ ಮೊತ್ತ | | ರೂ. 9,73,786/– |
| ಗುತ್ತಿಗೆದಾರರ ಹೆಸರು ಮತ್ತು ದರ್ಜೆ ಶ್ರೀ/ಮೆಸರ್ಸ್ | ಟೆಂಡರ್‌ನಲ್ಲಿ ಗುತ್ತಿಗೆದಾರರು ನಮೂದಿಸಿರುವ ದರಗಳಂತೆ ಟೆಂಡರಿನ ಮೊತ್ತ | ಮಂಜೂರಾದ ಅಂದಾಜಿನ ದರಗಳ ಮೇಲಿನ ಹಾಗೂ ಪರಿಷ್ಕರಿಸಿದ ದರಗಳ ಮೇಲಿನ ಶೇಕಡಾವಾರು ಹೆಚ್ಚಳ/ಕಡಿಮೆ |
| ಎ.ಎಂ. ಮುಲ್ಲಾ, ಒಂದನೇ ದರ್ಜೆ ಗುತ್ತಿಗೆದಾರರು | 11,21,733/– | 15.19 ಹೆಚ್ಚು |

ಮೇಲ್ಕಂಡಂತೆ ಶ್ರೀ ಎ.ಎಂ. ಮುಲ್ಲಾ, 1ನೇ ದರ್ಜೆ ಗುತ್ತಿಗೆದಾರರು ಇವರು ಟೆಂಡರ್‌ನಲ್ಲಿ ಅರ್ಹತೆ ಹೊಂದಿದ ಗುತ್ತಿಗೆದಾರರಾಗಿದ್ದು ಇವರು ನಮೂದಿಸಿದ ದರಗಳನ್ನು ಪ್ರಸಕ್ತ ಸಾಲಿನ ದರಗಳಿಗೆ ಪರಿಷ್ಕರಿಸಿದಂತೆ ಟೆಂಡರ್‌ಗಿಟ್ಟ ಮೊತ್ತಕ್ಕೆ ಹೋಲಿಸಿದಾಗ ಶೇಕಡ 15.19ರಷ್ಟು ಹೆಚ್ಚಾಗಿದ್ದು, ಸದರಿಯವರ ಟೆಂಡರನ್ನು ಸಂಧಾನದ ಮೂಲಕ ಅಂಗೀಕರಿಸಲು ಮುಖ್ಯ ಇಂಜಿನಿಯರ್, ಸಣ್ಣ ನೀರಾವರಿ ಉತ್ತರ ವಲಯ, ಬಿಜಾಪುರ ಇವರು ಮೇಲೆ ಓದಲಾದ ಪತ್ರದಲ್ಲಿ ಶಿಫಾರಸ್ಸು ಮಾಡಿರುತ್ತಾರೆ.

ಈ ಟೆಂಡರನ್ನು ಸರ್ಕಾರದಲ್ಲಿ ಪರಿಶೀಲಿಸಿ ಪ್ರಸಕ್ತ ಸಾಲಿನ ದರಗಳಿಗೆ ಪರಿಷ್ಕರಿಸಿದಂತೆ ಟೆಂಡರಿಗಿಟ್ಟ ಪರಿಷ್ಕೃತ ಮೊತ್ತ ರೂ. 9,73,786/– ಗಳ ಮೇಲೆ ಶೇಕಡಾ 14.00 ರಷ್ಟು ಹೆಚ್ಚಿನ ದರಗಳಿಗೆ ಅಂದರೆ ರೂ. 11,10,116/–ಗಳಿಗೆ ಟೆಂಡರನ್ನು ಅನುಮೋದಿಸಲು ಪರಿಗಣಿಸಿದೆ.

ಮೇಲಿನ ಅಂಶಗಳ ಹಿನ್ನೆಲೆಯಲ್ಲಿ ಸರ್ಕಾರವು ಈ ಕೆಳಕಂಡಂತೆ ಆದೇಶ ಹೊರಡಿಸಿದೆ.

**ಸರ್ಕಾರದ ಆದೇಶ ಸಂಖ್ಯೆ : ಸನೀಇ 85 ಏನೀಯೋ (ತಾಂತ್ರಿಕ) 2012, ಬೆಂಗಳೂರು, ದಿನಾಂಕ : 3ನೇ ಜನವರಿ, 2013.**

ಪ್ರಸ್ತಾವನೆಯಲ್ಲಿ ವಿವರಿಸಿರುವ ಅಂಶಗಳ ಹಿನ್ನೆಲೆಯಲ್ಲಿ ಬೆಳಗಾವಿ ಜಿಲ್ಲೆ ಚಿಕ್ಕೋಡಿ ತಾಲ್ಲೂಕಿನ ಅಕ್ಕೋಳ ಗ್ರಾಮದ ಹತ್ತಿರ ವೇದಗಂಗಾ ನದಿಯಿಂದ ಏತ ನೀರಾವರಿ ಯೋಜನೆ ನಿರ್ಮಾಣ ಕಾಮಗಾರಿಯನ್ನು ಪ್ರಸಕ್ತ ಸಾಲಿನ ದರಪಟ್ಟಿಯ ದರಗಳನ್ನು ಪರಿಗಣಿಸಿ ಪರಿಷ್ಕರಿಸಿದಂತೆ ಟೆಂಡರಿಗಿಡಲಾದ ಮೊತ್ತ ರೂ. 9,73,786/–ಗಳ ಮೇಲೆ ಶೇ. 14.00 ರಷ್ಟು ಹೆಚ್ಚಿನ ದರಗಳಿಗೆ ಅಂದರೆ ರೂ. 11,10,116/–ಗಳಿಗೆ (ರೂ. ಹನ್ನೊಂದು ಲಕ್ಷ ಹತ್ತು ಸಾವಿರದ ಒಂದು ನೂರ ಹದಿನಾರು ಮಾತ್ರ) ಗಳಿಗೆ ಶ್ರೀ ಎ.ಎಂ. ಮುಲ್ಲಾ, ಒಂದನೇ ದರ್ಜೆ ಗುತ್ತಿಗೆದಾರರು ರವರಿಗೆ ಕೆಳಕಂಡ ಷರತ್ತುಗಳಿಗೆ ಒಳಪಡಿಸಿ ವಹಿಸಲು ಸರ್ಕಾರವು ಅನುಮೋದನೆ ನೀಡಿದೆ.

1. ಕಾಮಗಾರಿಯನ್ನು ನಿಗದಿತ ಅವಧಿಯಲ್ಲಿ ಪೂರ್ಣಗೊಳಿಸತಕ್ಕದ್ದು.
2. ಸರ್ಕಾರದ ಅನುಮತಿ ಪಡೆಯದೆ ಕಾಮಗಾರಿಯಲ್ಲಿ ಯಾವುದೇ ಹೆಚ್ಚುವರಿ ಕೆಲಸ ನಿರ್ವಹಿಸಬಾರದು.

ಈ ಆದೇಶವನ್ನು ಆರ್ಥಿಕ ಇಲಾಖೆಯ ಆದೇಶ ಸಂಖ್ಯೆ : ಎಫ್‌ಡಿ 1 ಟಿಎಫ್‌ಪಿ 2002, ದಿನಾಂಕ : 20–1–2003 ರಲ್ಲಿ ಇಲಾಖಾ ಕಾರ್ಯದರ್ಶಿಯವರಿಗೆ ನೀಡಿರುವ ಆರ್ಥಿಕಾಧಿಕಾರದನ್ವಯ ಹೊರಡಿಸಲಾಗಿದೆ.

ಕರ್ನಾಟಕ ರಾಜ್ಯಪಾಲರ ಆದೇಶಾನುಸಾರ ಮತ್ತು ಅವರ ಹೆಸರಿನಲ್ಲಿ
**ರುದ್ರಮೂರ್ತಿ**
ಪದನಿಮಿತ್ತ ಸರ್ಕಾರದ ಅಧೀನ ಕಾರ್ಯದರ್ಶಿ,
ಜಲಸಂಪನ್ಮೂಲ ಇಲಾಖೆ (ಸಣ್ಣ ನೀರಾವರಿ).

P.R. 100

## ಜಲಸಂಪನ್ಮೂಲ ಸಚಿವಾಲಯ

**ವಿಷಯ :** ಬಿಜಾಪುರ ಜಿಲ್ಲೆ ಹಾಗೂ ತಾಲ್ಲೂಕಿನ ಕಾರಜೋಳ ಗ್ರಾಮದ ಹತ್ತಿರ ಏತ ನೀರಾವರಿ ಯೋಜನೆ ನಿರ್ಮಾಣ ಕಾಮಗಾರಿಯ ಟೆಂಡರ್ ಅನುಮೋದಿಸುವ ಬಗ್ಗೆ.

**ಓದಲಾಗಿದೆ :**
1. ಸರ್ಕಾರದ ಆದೇಶ ಸಂಖ್ಯೆ : ಸನೀಇ 61 ಏನೀಯೋ 2012, ದಿನಾಂಕ : 17–8–2012.
2. ಮುಖ್ಯ ಇಂಜಿನಿಯರ್, ಸಣ್ಣ ನೀರಾವರಿ ಉತ್ತರ ವಲಯ ಬಿಜಾಪುರರವರ ಪತ್ರದ ಕ್ರಮಾಂಕ : ಮುಇಂ/ಸನೀ(ಉ) ವಲಯ/ಬಿಜೆಪಿ/ಪಿಬಿ–9/ಕಾರಜೋಳ ಏನೀಯೋ/2012–13/6471, ದಿನಾಂಕ : 29–11–2012.
3. ದಿನಾಂಕ : 3–12–2012 ರಂದು ನಡೆದ ಇಲಾಖಾ ಟೆಂಡರ್ ಪರಿಶೀಲನಾ ಸಮಿತಿಯ ಸಭೆಯ ನಡವಳಿ.

**ಪ್ರಸ್ತಾವನೆ :**

ಬಿಜಾಪುರ ಜಿಲ್ಲೆ ಹಾಗೂ ತಾಲ್ಲೂಕಿನ ಕಾರಜೋಳ ಗ್ರಾಮದ ಹತ್ತಿರ ಏತ ನೀರಾವರಿ ಯೋಜನೆ ನಿರ್ಮಾಣ ಕಾಮಗಾರಿ ಅಂದಾಜಿಗೆ ಉಲ್ಲೇಖ (1) ರಲ್ಲಿ ನಮೂದಿಸಿರುವ ಸರ್ಕಾರದ ಆದೇಶದಲ್ಲಿ ರೂ. 8465.00 ಲಕ್ಷಗಳಿಗೆ ಆಡಳಿತಾತ್ಮಕ ಅನುಮೋದನೆ ನೀಡಲಾಗಿದ್ದು ಮುಖ್ಯ ಇಂಜಿನಿಯರ್, ಸಣ್ಣ ನೀರಾವರಿ ಉತ್ತರ ವಲಯ ಬಿಜಾಪುರರವರು ತಾಂತ್ರಿಕ ಮಂಜೂರಾತಿ ನೀಡಿರುತ್ತಾರೆ.

ಈ ಕಾಮಗಾರಿಯನ್ನು ಕೈಗೊಳ್ಳಲು ಬಿಜಾಪುರ ಸಣ್ಣ ನೀರಾವರಿ ವಿಭಾಗದಿಂದ ಕರ್ನಾಟಕ ಸಾರ್ವಜನಿಕ ಸಂಗ್ರಹಣೆಗಳಲ್ಲಿ ಪಾರದರ್ಶಕತೆ ಅಧಿನಿಯಮದಡಿ ಇ–ಪ್ರೊಕ್ಯೂರ್‌ಮೆಂಟ್ ಮೂಲಕ ಕರೆಯಲಾದ ಟೆಂಡರ್ ಪ್ರಕಟಣೆಯನ್ನು ಕೆಳಕಂಡ ಮಾಧ್ಯಮಗಳಲ್ಲಿ ಪ್ರಕಟಿಸಲಾಗಿದೆ.

| | |
|---|---|
| ರಾಜ್ಯ ಟೆಂಡರ್ ಬುಲೆಟಿನ್ | 22–9–2012 |
| ಇಂಡಿಯನ್ ಟ್ರೇಡ್ ಜರ್ನಲ್ | 26–9–2012 |
| ವಿಜಯ ಕರ್ನಾಟಕ ದಿನ ಪತ್ರಿಕೆ | 19–9–2012 |
| ಪ್ರಜಾವಾಣಿ ದಿನ ಪತ್ರಿಕೆ | 19–9–2012 |
| ಟೈಮ್ಸ್ ಆಫ್ ಇಂಡಿಯಾ ದಿನ ಪತ್ರಿಕೆ | 19–9–2012 |

ದಿನಾಂಕ : 6–11–2012 ರಂದು ಇ–ಪ್ರೊಕ್ಯೂರ್‌ಮೆಂಟ್ ಮೂಲಕ ತಾಂತ್ರಿಕ ಬಿಡ್ ಅನ್ನು ತೆರೆದು ಪರಿಶೀಲಿಸಲಾಗಿರುತ್ತದೆ. ಈ ಟೆಂಡರ್ ಪ್ರಕಟಣೆಗೆ ಸ್ಪಂದಿಸಿ ಇಬ್ಬರು ಗುತ್ತಿಗೆದಾರರು ಭಾಗವಹಿಸಿದ್ದು ಇವರು ಅರ್ಹತೆ ಹೊಂದಿರುತ್ತಾರೆ. ಇವರ ಆರ್ಥಿಕ ಬಿಡ್ ಅನ್ನು ದಿನಾಂಕ : 22–11–2012 ರಂದು ತೆರೆಯಲಾಗಿದ್ದು ವಿವರಗಳು ಕೆಳಕಂಡಂತಿವೆ.

| | | | |
|---|---|---|---|
| ಮಂಜೂರಾದ ಅಂದಾಜಿನ ದರಗಳಂತೆ ಟೆಂಡರಿಗೆ ಇಡಲಾದ ಮೊತ್ತ | | ರೂ. 78,32,73,940/– | |
| ಪ್ರಸಕ್ತ ಸಾಲಿನ ದರಗಳನ್ನು ಪರಿಗಣಿಸಿ ಪರಿಷ್ಕರಿಸಿದಂತೆ ಟೆಂಡರಿಗೆ ಇಡಲಾದ ಮೊತ್ತ | | ರೂ. 89,08,02,982/– | |
| ಗುತ್ತಿಗೆದಾರರ ಹೆಸರು ಮತ್ತು ದರ್ಜೆ ಶ್ರೀ/ಮೆಸರ್ಸ್ | ಟೆಂಡರ್‌ನಲ್ಲಿ ಗುತ್ತಿಗೆದಾರರು ನಮೂದಿಸಿರುವ ದರಗಳಂತೆ ಟೆಂಡರಿನ ಮೊತ್ತ | ಮಂಜೂರಾದ ಅಂದಾಜಿನ ದರಗಳ ಮೇಲಿನ ಶೇಕಡಾವಾರು ಹೆಚ್ಚಳ/ಕಡಿಮೆ | ಪರಿಷ್ಕರಿಸಿದ ದರಗಳ ಮೇಲಿನ ಶೇಕಡಾವಾರು ಹೆಚ್ಚಳ/ಕಡಿಮೆ |
| ಜಿ. ಶಂಕರ, ಒಂದನೇ ದರ್ಜೆ ಗುತ್ತಿಗೆದಾರರು | 1,11,75,17,888/– | 42.87 ಹೆಚ್ಚು | 25.45 ಹೆಚ್ಚು |
| ಮೆ: ಕಿರ್ಲೋಸ್ಕರ್ ಬ್ರದರ್ಸ್ ಲಿ. ಟಿ.ವಿ. ಸುಧೀರ್ ಮೋಹನ್, ಒಂದನೇ ದರ್ಜೆ ಗುತ್ತಿಗೆದಾರರು | 1,20,40,95,467/– | 53.72 ಹೆಚ್ಚು | 35.17 ಹೆಚ್ಚು |

ಮೇಲ್ಕಂಡಂತೆ ಶ್ರೀ ಜಿ. ಶಂಕರ, ಒಂದನೇ ದರ್ಜೆ ಗುತ್ತಿಗೆದಾರರು ಇವರು ಟೆಂಡರ್‌ನಲ್ಲಿ ಅರ್ಹತೆ ಹೊಂದಿರುವ ಗುತ್ತಿಗೆದಾರರಾಗಿದ್ದು ಇವರು ನಮೂದಿಸಿದ ದರಗಳನ್ನು ಪ್ರಸಕ್ತ ಸಾಲಿನ ದರಗಳಿಗೆ ಪರಿಷ್ಕರಿಸಿದ ಟೆಂಡರ್‌ಗಿಟ್ಟ ಮೊತ್ತಕ್ಕೆ ಹೋಲಿಸಿದಾಗ ಶೇಕಡ 25.45ರಷ್ಟು ಹೆಚ್ಚಾಗಿರುತ್ತದೆ. ಸದರಿ ಟೆಂಡರನ್ನು ದಿನಾಂಕ : 3–12–2012 ರಂದು ನಡೆದ ಇಲಾಖಾ ಟೆಂಡರ್ ಪರಿಶೀಲನಾ ಸಮಿತಿ ಸಭೆಯ ಮುಂದೆ ಮಂಡಿಸಲಾಯಿತು. ಸಮಿತಿಯು ಕೆಳಕಂಡಂತೆ ಶಿಫಾರಸ್ಸು ಮಾಡಿರುತ್ತದೆ.

"ಗುತ್ತಿಗೆದಾರರು ಮನವಿ ಮಾಡಿದ ಅಂಶಗಳನ್ನು ಸಭೆಯಲ್ಲಿ ಚರ್ಚಿಸಲಾಯಿತು. ಪ್ರಸಕ್ತ ಸಾಲಿನ ದರಪಟ್ಟಿಯ ದರಗಳಿಗೆ ಪರಿಷ್ಕರಿಸಿದಂತೆ ಟೆಂಡರಿಗೆ ಇಡಲಾದ ಮೊತ್ತ ರೂ. 89,08,02,982/– ಗಳ ಮೇಲೆ ಶೇ. 15.00 ರಷ್ಟು ಹೆಚ್ಚಿನ ಮೊತ್ತಕ್ಕೆ ಅಂದರೆ ರೂ. 102,44,23,429/–ಗಳಿಗೆ ಶ್ರೀ ಜಿ. ಶಂಕರ, ಇವರ ಟೆಂಡರನ್ನು ಅನುಮೋದಿಸುವಂತೆ ಸರ್ಕಾರಕ್ಕೆ ಶಿಫಾರಸ್ಸು ಮಾಡಲು ತೀರ್ಮಾನಿಸಲಾಯಿತು.

ಈ ಟೆಂಡರನ್ನು ಸರ್ಕಾರದಲ್ಲಿ ಪರಿಶೀಲಿಸಿ ಪ್ರಸಕ್ತ ಸಾಲಿನ ದರಗಳಿಗೆ ಪರಿಷ್ಕರಿಸಿದಂತೆ ಟೆಂಡರಿಗಿಟ್ಟ ಪರಿಷ್ಕೃತ ಮೊತ್ತ ರೂ. 89,08,02,982/– ಗಳ ಮೇಲೆ ಶೇಕಡಾ 14.95 ರಷ್ಟು ಹೆಚ್ಚಿನ ದರಗಳಿಗೆ ಅಂದರೆ ರೂ. 1,02,39,78,028/–ಗಳಿಗೆ ಟೆಂಡರನ್ನು ಅನುಮೋದಿಸಲು ಪರಿಗಣಿಸಿದೆ.

ಮೇಲಿನ ಅಂಶಗಳ ಹಿನ್ನೆಲೆಯಲ್ಲಿ ಸರ್ಕಾರವು ಈ ಕೆಳಕಂಡಂತೆ ಆದೇಶ ಹೊರಡಿಸಿದೆ.

**ಸರ್ಕಾರದ ಆದೇಶ ಸಂಖ್ಯೆ : ಸನೀಇ 88 ಏನೀಯೋ (ತಾಂತ್ರಿಕ) 2012, ಬೆಂಗಳೂರು, ದಿನಾಂಕ : 14ನೇ ಡಿಸೆಂಬರ್, 2012.**

ಪ್ರಸ್ತಾವನೆಯಲ್ಲಿ ವಿವರಿಸಿರುವ ಅಂಶಗಳ ಹಿನ್ನೆಲೆಯಲ್ಲಿ ಬಿಜಾಪುರ ಜಿಲ್ಲೆ ಹಾಗೂ ತಾಲ್ಲೂಕಿನ ಕಾರಜೋಳ ಗ್ರಾಮದ ಹತ್ತಿರ ಏತ ನೀರಾವರಿ ಯೋಜನೆ ನಿರ್ಮಾಣ ಕಾಮಗಾರಿಯನ್ನು ಪ್ರಸಕ್ತ ಸಾಲಿನ ದರಪಟ್ಟಿಯ ದರಗಳನ್ನು ಪರಿಗಣಿಸಿ ಪರಿಷ್ಕರಿಸಿದಂತೆ ಟೆಂಡರಿಗಿಡಲಾದ ಮೊತ್ತ ರೂ. 89,08,02,982/–ಗಳ ಮೇಲೆ ಶೇ. 14.95ರಷ್ಟು ಹೆಚ್ಚಿನ ದರಗಳಿಗೆ ಅಂದರೆ ರೂ. 1,02,39,78,028/–ಗಳಿಗೆ (ರೂ. ಒಂದುನೂರ ಎರಡು ಕೋಟಿ ಮೂವತ್ತೊಂಬತ್ತು ಲಕ್ಷ ಎಪ್ಪತ್ತೆಂಟು ಸಾವಿರದ ಇಪ್ಪತ್ತೆಂಟು ಮಾತ್ರ) ಗಳಿಗೆ ಶ್ರೀ ಜಿ. ಶಂಕರ, ಒಂದನೇ ದರ್ಜೆ ಗುತ್ತಿಗೆದಾರರು ರವರಿಗೆ ಕೆಳಕಂಡ ಷರತ್ತುಗಳಿಗೆ ಒಳಪಡಿಸಿ ವಹಿಸಲು ಸರ್ಕಾರವು ಅನುಮೋದನೆ ನೀಡಿದೆ.

1. ಕಾಮಗಾರಿಯನ್ನು ನಿಗಧಿತ ಅವಧಿಯಲ್ಲಿ ಪೂರ್ಣಗೊಳಿಸತಕ್ಕದ್ದು.
2. ಸರ್ಕಾರದ ಅನುಮತಿ ಪಡೆಯದೆ ಕಾಮಗಾರಿಯಲ್ಲಿ ಯಾವುದೇ ಹೆಚ್ಚುವರಿ ಕೆಲಸ ನಿರ್ವಹಿಸಬಾರದು.

ಈ ಆದೇಶವನ್ನು ಆರ್ಥಿಕ ಇಲಾಖೆಯ ಆದೇಶ ಸಂಖ್ಯೆ : ಎಫ್‌ಡಿ 1 ಟಿಎಫ್‌ಪಿ 2002, ದಿನಾಂಕ : 20–1–2003 ರಲ್ಲಿ ಇಲಾಖಾ ಕಾರ್ಯದರ್ಶಿಯವರಿಗೆ ನೀಡಿರುವ ಆರ್ಥಿಕಾಧಿಕಾರದನ್ವಯ ಹೊರಡಿಸಲಾಗಿದೆ.

ಕರ್ನಾಟಕ ರಾಜ್ಯಪಾಲರ ಆದೇಶಾನುಸಾರ ಮತ್ತು ಅವರ ಹೆಸರಿನಲ್ಲಿ

**ರುದ್ರಮೂರ್ತಿ**

ಪದನಿಮಿತ್ತ ಸರ್ಕಾರದ ಅಧೀನ ಕಾರ್ಯದರ್ಶಿ,

ಜಲಸಂಪನ್ಮೂಲ ಇಲಾಖೆ (ಸಣ್ಣ ನೀರಾವರಿ).

P.R. 2262

## ಜಲಸಂಪನ್ಮೂಲ ಸಚಿವಾಲಯ

**ವಿಷಯ :** ಬಾಗಲಕೋಟೆ ಜಿಲ್ಲೆ ಹಾಗೂ ತಾಲ್ಲೂಕಿನ ಮುಗಳೊಳ್ಳಿ ಗ್ರಾಮದ ಹತ್ತಿರ ಏತ ನೀರಾವರಿ ಯೋಜನೆ ರೈಸಿಂಗ್ ಮೇನ್ ಅನ್ನು ರೈಲ್ವೆ ಕ್ರಾಸಿಂಗ್‌ನಲ್ಲಿ ಪೈಪ್ ಲೈನ್ ಮೂಲಕ ಅಳವಡಿಸುವ ಬಗ್ಗೆ.

**ಓದಲಾಗಿದೆ :**

1. ಸರ್ಕಾರದ ಆದೇಶ ಸಂಖ್ಯೆ : ಸನೀಇ 10 ನಯೋಕಾ 2010, ದಿನಾಂಕ : 20–10–2010
2. ಮುಖ್ಯ ಇಂಜಿನಿಯರ್, ಸಣ್ಣ ನೀರಾವರಿ ಉತ್ತರ ವಲಯ ಬಿಜಾಪುರರವರ ಪತ್ರದ ಸಂಖ್ಯೆ: ಮುಇಂ/ಸನೀ(ಉ)ವಲಯ/ಬಿಜೆಪಿ/ಎಇ–6/2012–13/6403, ದಿನಾಂಕ : 26–10–2012

**ಪ್ರಸ್ತಾವನೆ :**

ಬಾಗಲಕೋಟೆ ಜಿಲ್ಲೆ ಹಾಗೂ ತಾಲ್ಲೂಕಿನ ಮುಗಳೊಳ್ಳಿ ಗ್ರಾಮದ ಹತ್ತಿರ ಏತ ನೀರಾವರಿ ಯೋಜನೆಯ ಕಾಮಗಾರಿ ಅಂದಾಜಿಗೆ ಉಲ್ಲೇಖ (1) ರಲ್ಲಿ ನಮೂದಿಸಿರುವ ಸರ್ಕಾರದ ಆದೇಶದಲ್ಲಿ ರೂ. 1854.00 ಲಕ್ಷಗಳಿಗೆ ಆಡಳಿತಾತ್ಮಕ ಅನುಮೋದನೆ ನೀಡಲಾಗಿದ್ದು ಮುಖ್ಯ ಇಂಜಿನಿಯರ್, ಸಣ್ಣ ನೀರಾವರಿ ಉತ್ತರ ವಲಯ ಬಿಜಾಪುರರವರು ತಾಂತ್ರಿಕ ಮಂಜೂರಾತಿ ನೀಡಿರುತ್ತಾರೆ.

ಈ ಕಾಮಗಾರಿಯಲ್ಲಿ ರೈಲ್ವೆ ಹಳಿ ಹಾದುಹೋಗುವ ಕಾಮಗಾರಿ ಇದ್ದು ಈ ಭಾಗದ ಕಾಮಗಾರಿಯನ್ನು ಹೊರತುಪಡಿಸಿ ಉಳಿದ ಕಾಮಗಾರಿಯನ್ನು ಟೆಂಡರ್ ಆಧಾರದ ಮೇಲೆ ಕೈಗೊಳ್ಳಲಾಗಿದ್ದು ಇದು ಮುಕ್ತಾಯದ ಹಂತದಲ್ಲಿರುತ್ತದೆ. ರೈಲ್ವೆ ಕ್ರಾಸಿಂಗ್‌ನಲ್ಲಿ ರೈಸಿಂಗ್‌ಮೇನ್ ಅನ್ನು ಪೈಪ್ ಲೈನ್ ಮೂಲಕ ಅಳವಡಿಸುವ ಕಾಮಗಾರಿಗೆ ರೂ. 52.30 ಲಕ್ಷ ಮೊತ್ತಕ್ಕೆ ಒಂದು ಪ್ರತ್ಯೇಕವಾದ ಅಂದಾಜನ್ನು ತಯಾರಿಸಲಾಗಿದ್ದು ಇದಕ್ಕೆ ತಾಂತ್ರಿಕ ಅನುಮೋದನೆ ನೀಡಲಾಗಿರುತ್ತದೆ. ಈ ಕಾಮಗಾರಿಯನ್ನು ಕೈಗೊಳ್ಳಲು ಈಗ ಪ್ರತ್ಯೇಕವಾಗಿ ಟೆಂಡರನ್ನು ಕರೆಯಲಾಗಿರುತ್ತದೆ.

| | |
|---|---|
| ಜಿಲ್ಲಾ ಟೆಂಡರ್ ಬುಲೆಟಿನ್ | 6–10–2012 |
| ಪ್ರಜಾವಾಣಿ ದಿನ ಪತ್ರಿಕೆ | 6–10–2012 |
| ಕನ್ನಡ ಪ್ರಭ ದಿನ ಪತ್ರಿಕೆ | 6–10–2012 |

ದಿನಾಂಕ : 26–10–2012 ರಂದು ಇ–ಪ್ರೊಕ್ಯೂರ್‌ಮೆಂಟ್ ಮೂಲಕ ಟೆಂಡರನ್ನು ತೆರೆದು ಪರಿಶೀಲಿಸಲಾಗಿರುತ್ತದೆ. ಈ ಟೆಂಡರ್ ಪ್ರಕಟಣೆಗೆ ಸ್ಪಂದಿಸಿ ಒಬ್ಬರು ಗುತ್ತಿಗೆದಾರರು ಮಾತ್ರ ಭಾಗವಹಿಸಿದ್ದು ಇವರು ಅರ್ಹತೆ ಹೊಂದಿರುತ್ತಾರೆ. ವಿವರಗಳು ಕೆಳಕಂಡಂತಿವೆ.

| | | |
|---|---|---|
| ಮಂಜೂರಾದ ಅಂದಾಜಿನ ದರಗಳಂತೆ ಹಾಗೂ ಪ್ರಸಕ್ತ ಸಾಲಿನ ದರಗಳನ್ನು ಪರಿಗಣಿಸಿ ಪರಿಷ್ಕರಿಸಿದಂತೆ ಟೆಂಡರಿಗೆ ಇಡಲಾದ ಮೊತ್ತ | | ರೂ. 38,56,808/– |
| ಗುತ್ತಿಗೆದಾರರ ಹೆಸರು ಮತ್ತು ದರ್ಜೆ ಶ್ರೀ/ಮೆಸರ್ಸ್ | ಟೆಂಡರ್‌ನಲ್ಲಿ ಗುತ್ತಿಗೆದಾರರು ನಮೂದಿಸಿರುವ ದರಗಳಂತೆ ಟೆಂಡರಿನ ಮೊತ್ತ | ಮಂಜೂರಾದ ಅಂದಾಜಿನ ದರಗಳ ಮೇಲಿನ ಹೆಚ್ಚಳ/ಕಡಿಮೆ ಪರಿಷ್ಕರಿಸಿದ ದರಗಳ ಮೇಲಿನ ಶೇಕಡಾವಾರು ಹೆಚ್ಚಳ/ಕಡಿಮೆ |
| ಮೆ: ತಾನ್ಯಾ ಅಸೋಸಿಯೇಟ್ಸ್ (ಸುಧಾ ಗುರುರಾಜನ್) ಒಂದನೇ ದರ್ಜೆ ಗುತ್ತಿಗೆದಾರರು | 49,00,000/– | 27.05 ಹೆಚ್ಚು |

ಮೇಲ್ಕಂಡಂತೆ ಮೆ: ತಾನ್ಯಾ ಅಸೋಸಿಯೇಟ್ಸ್ (ಸುಧಾ ಗುರುರಾಜನ್) ಒಂದನೇ ದರ್ಜೆ ಗುತ್ತಿಗೆದಾರರು ಇವರು ಟೆಂಡರ್‌ನಲ್ಲಿ ಅರ್ಹತೆ ಹೊಂದಿದ ಗುತ್ತಿಗೆದಾರರಾಗಿದ್ದು ಇವರು ನಮೂದಿಸಿದ ದರಗಳನ್ನು ಪ್ರಸಕ್ತ ಸಾಲಿನ ದರಗಳಿಗೆ ಪರಿಷ್ಕರಿಸಿದಂತೆ ಟೆಂಡರ್‌ಗಿಟ್ಟ ಮೊತ್ತಕ್ಕೆ ಹೋಲಿಸಿದಾಗ ಶೇಕಡ 27.05ರಷ್ಟು ಹೆಚ್ಚಾಗಿದ್ದು, ಸದರಿಯವರ ಟೆಂಡರನ್ನು ಸಂಧಾನದ ಮೂಲಕ ಅಂಗೀಕರಿಸಲು ಮುಖ್ಯ ಇಂಜಿನಿಯರ್, ಸಣ್ಣ ನೀರಾವರಿ ಉತ್ತರ ವಲಯ, ಬಿಜಾಪುರ ಇವರು ಮೇಲೆ ಓದಲಾದ ಪತ್ರದಲ್ಲಿ ಶಿಫಾರಸ್ಸು ಮಾಡಿರುತ್ತಾರೆ.

ಈ ಟೆಂಡರನ್ನು ಸರ್ಕಾರದಲ್ಲಿ ಪರಿಶೀಲಿಸಿ ಪ್ರಸಕ್ತ ಸಾಲಿನ ದರಗಳಿಗೆ ಪರಿಷ್ಕರಿಸಿದಂತೆ ಟೆಂಡರಿಗಿಟ್ಟ ಪರಿಷ್ಕೃತ ಮೊತ್ತ ರೂ. 38,56,808/– ಗಳ ಮೇಲೆ ಶೇಕಡಾ 14.50 ರಷ್ಟು ಹೆಚ್ಚಿನ ದರಗಳಿಗೆ ಅಂದರೆ ರೂ. 44,16,045/–ಗಳಿಗೆ ಟೆಂಡರನ್ನು ಅನುಮೋದಿಸಲು ಪರಿಗಣಿಸಿದೆ.

ಮೇಲಿನ ಅಂಶಗಳ ಹಿನ್ನೆಲೆಯಲ್ಲಿ ಸರ್ಕಾರವು ಈ ಕೆಳಕಂಡಂತೆ ಆದೇಶ ಹೊರಡಿಸಿದೆ.

**ಸರ್ಕಾರದ ಆದೇಶ ಸಂಖ್ಯೆ : ಸನೀಇ 89 ಏನೀಯೋ (ತಾಂತ್ರಿಕ) 2012, ಬೆಂಗಳೂರು, ದಿನಾಂಕ : 4ನೇ ಡಿಸೆಂಬರ್, 2012.**

ಪ್ರಸ್ತಾವನೆಯಲ್ಲಿ ವಿವರಿಸಿರುವ ಅಂಶಗಳ ಹಿನ್ನೆಲೆಯಲ್ಲಿ ಬಾಗಲಕೋಟೆ ಜಿಲ್ಲೆ ಹಾಗೂ ತಾಲ್ಲೂಕಿನ ಮುಗಳೊಳ್ಳಿ ಗ್ರಾಮದ ಹತ್ತಿರ ಏತ ನೀರಾವರಿ ಯೋಜನೆ ರೈಸಿಂಗ್ ಮೇನ್ ಅನ್ನು ರೈಲ್ವೆ ಕ್ರಾಸಿಂಗ್‌ನಲ್ಲಿ ಪೈಪ್ ಲೈನ್ ಮೂಲಕ ಅಳವಡಿಸುವ ಕಾಮಗಾರಿಯನ್ನು ಪ್ರಸಕ್ತ ಸಾಲಿನ ದರಪಟ್ಟಿಯ ದರಗಳನ್ನು ಪರಿಗಣಿಸಿ ಪರಿಷ್ಕರಿಸಿದಂತೆ ಟೆಂಡರಿಗಿಡಲಾದ ಮೊತ್ತ ರೂ. 38,56,808/–ಗಳ ಮೇಲೆ ಶೇ. 14.50ರಷ್ಟು ಹೆಚ್ಚಿನ ದರಗಳಿಗೆ ಅಂದರೆ ರೂ. 44,16,045/– ಗಳಿಗೆ (ರೂ. ನಲವತ್ತನಾಲ್ಕು ಲಕ್ಷ ಹದಿನಾರು ಸಾವಿರದ ನಲವತ್ತೈದು ಮಾತ್ರ) ಗಳಿಗೆ ಮೆ: ತಾನ್ಯಾ ಅಸೋಸಿಯೇಟ್ಸ್ (ಸುಧಾ ಗುರುರಾಜನ್), ಒಂದನೇ ದರ್ಜೆ ಗುತ್ತಿಗೆದಾರರು ರವರಿಗೆ ಕೆಳಕಂಡ ಷರತ್ತುಗಳಿಗೆ ಒಳಪಡಿಸಿ ವಹಿಸಲು ಸರ್ಕಾರವು ಅನುಮೋದನೆ ನೀಡಿದೆ.

1. ಕಾಮಗಾರಿಯನ್ನು ನಿಗದಿತ ಅವಧಿಯಲ್ಲಿ ಪೂರ್ಣಗೊಳಿಸತಕ್ಕದ್ದು.
2. ಸರ್ಕಾರದ ಅನುಮತಿ ಪಡೆಯದೆ ಕಾಮಗಾರಿಯಲ್ಲಿ ಯಾವುದೇ ಹೆಚ್ಚುವರಿ ಕೆಲಸ ನಿರ್ವಹಿಸಬಾರದು.

ಈ ಆದೇಶವನ್ನು ಆರ್ಥಿಕ ಇಲಾಖೆಯ ಆದೇಶ ಸಂಖ್ಯೆ : ಎಫ್‌ಡಿ 1 ಟಿಎಫ್‌ಪಿ 2002, ದಿನಾಂಕ : 20–1–2003 ರಲ್ಲಿ ಇಲಾಖಾ ಕಾರ್ಯದರ್ಶಿಯವರಿಗೆ ನೀಡಿರುವ ಆರ್ಥಿಕಾಧಿಕಾರದನ್ವಯ ಹೊರಡಿಸಲಾಗಿದೆ.

ಕರ್ನಾಟಕ ರಾಜ್ಯಪಾಲರ ಆದೇಶಾನುಸಾರ ಮತ್ತು ಅವರ ಹೆಸರಿನಲ್ಲಿ

**ರುದ್ರಮೂರ್ತಿ**

ಪದನಿಮಿತ್ತ ಸರ್ಕಾರದ ಅಧೀನ ಕಾರ್ಯದರ್ಶಿ,

**P.R. 2253** ಜಲಸಂಪನ್ಮೂಲ ಇಲಾಖೆ (ಸಣ್ಣ ನೀರಾವರಿ).

## ಜಲಸಂಪನ್ಮೂಲ ಸಚಿವಾಲಯ

**ವಿಷಯ :** ಬಾಗಲಕೋಟೆ ಜಿಲ್ಲೆ ಹುನಗುಂದ ತಾಲ್ಲೂಕು ಹುನಗುಂದ ಪಟ್ಟಣದ ಹತ್ತಿರ ಹಿರೇಹಳ್ಳಕ್ಕೆ ಬ್ರಿಡ್ಜ್ ಕಂ ಬ್ಯಾರೇಜ್ ನೀರಾವರಿ ಕಾಮಗಾರಿಯ ಅಂದಾಜಿಗೆ ಆಡಳಿತಾತ್ಮಕ ಅನುಮೋದನೆ ನೀಡುವ ಬಗ್ಗೆ.

**ಓದಲಾಗಿದೆ :** ಮುಖ್ಯ ಇಂಜಿನಿಯರ್, ಸಣ್ಣ ನೀರಾವರಿ ಉತ್ತರ ವಲಯ ಬಿಜಾಪುರರವರ ಪತ್ರದ ಸಂಖ್ಯೆ: ಮುಇಂ/ಸನೀ(ಉ)ವಲಯ/ಬಿಜೆಪಿ/ಎಇ–6/2011–12/4628, ದಿನಾಂಕ : 14–8–2012

**ಪ್ರಸ್ತಾವನೆ :**

ಬಾಗಲಕೋಟೆ ಜಿಲ್ಲೆ ಹುನಗುಂದ ತಾಲ್ಲೂಕು ಹುನಗುಂದ ಪಟ್ಟಣದ ಹತ್ತಿರ ಹಿರೇಹಳ್ಳಕ್ಕೆ ಅಡ್ಡಲಾಗಿ ಬ್ರಿಡ್ಜ್ ಕಂ ಬ್ಯಾರೇಜ್ ನಿರ್ಮಾಣ ಕಾಮಗಾರಿಯ 2012–13ನೇ ಸಾಲಿಗೆ ಮುಂದುವರೆಸಲಾದ 2010–11ನೇ ಸಾಲಿನ ದರಪಟ್ಟಿಯ ದರಗಳನ್ನಳವಡಿಸಿ ಸಿದ್ಧಪಡಿಸಿರುವ ರೂ. 297.50 ಲಕ್ಷ ಅಂದಾಜು ಪಟ್ಟಿಗೆ ಆಡಳಿತಾತ್ಮಕ ಅನುಮೋದನೆ ಕೋರಿ ಮೇಲೆ ಓದಲಾದ ಪತ್ರದೊಂದಿಗೆ ಮುಖ್ಯ ಇಂಜಿನಿಯರ್, ಸಣ್ಣ ನೀರಾವರಿ ಉತ್ತರ ವಲಯ ಬಿಜಾಪುರರವರು ಪ್ರಸ್ತಾವನೆ ಸಲ್ಲಿಸಿರುತ್ತಾರೆ.

ಉದ್ದೇಶಿತ ಬ್ಯಾರೇಜಿನ ಉದ್ದ–74.00 ಮೀ ಮೇಲ್ಭಾಗದಲ್ಲಿ 4.60 ಮೀ ಅಗಲ, ಮತ್ತು ಎತ್ತರ 2.50 ಮೀಗಳಾಗಿದ್ದು 14 ಮುಖ್ಯ ನಡುಗಂಬಗಳು ಹಾಗೂ 15 ನೆಪಮಾತ್ರ ನಡುಗಂಬಗಳು ಮತ್ತು 30 ಕಿಂಡಿಗಳೊಂದಿಗೆ ನಿರ್ಮಿಸಲು ವಿನ್ಯಾಸಿಸಲಾಗಿರುತ್ತದೆ. ನೀರಿನ ಶೇಖರಣಾ ಸಾಮರ್ಥ್ಯವು 10.96 ದಶಲಕ್ಷ ಘನ ಅಡಿಗಳಾಗಿದ್ದು ಈ ಯೋಜನೆಯ ನಿರ್ಮಾಣದಿಂದ 90 ಹೆಕ್ಟೇರ್ ಪ್ರದೇಶಕ್ಕೆ ನೀರಾವರಿ ಸೌಲಭ್ಯ ಕಲ್ಪಿಸಲು ಉದ್ದೇಶಿಸಲಾಗಿದೆ. ಈ ಯೋಜನೆಯ ಲಾಭ ವೆಚ್ಚದ ಅನುಪಾತ ಶೇಕಡಾ 10ರ ದರದಲ್ಲಿ 1.26 ಆಗಿದ್ದು ಆರ್ಥಿಕವಾಗಿ ಶಕ್ಯವಾಗಿರುತ್ತದೆ.

ಈ ಕಾಮಗಾರಿಯ ಅಂದಾಜನ್ನು ದಿನಾಂಕ : 13–7–2012ರಂದು ನಡೆದ ತಾಂತ್ರಿಕ ಮೌಲ್ಯ ನಿರ್ಣಯ ಸಮಿತಿ ಸಭೆಯ ಮುಂದೆ ಮಂಡಿಸಲಾಗಿದ್ದು ಸಮಿತಿಯು ಕೆಲವು ಷರಾಗಳೊಂದಿಗೆ ತೀರುವಳಿ ನೀಡಿರುತ್ತದೆ.

2012–13ನೇ ಸಾಲಿನ ಅಪೆಂಡಿಕ್ಸ್–ಇ ಲೆಕ್ಕ ಶೀರ್ಷಿಕೆ "4702–00–101–5–01–139 ಅಣೆಕಟ್ಟು ಮತ್ತು ಪಿಕಪ್–ಪ್ರಧಾನ ಕಾಮಗಾರಿಗಳು" ರಡಿಯಲ್ಲಿ ರೂ. 300.00 ಲಕ್ಷ ಅಂದಾಜು ಮೊತ್ತ ಹಾಗೂ ರೂ. 100.00 ಲಕ್ಷಗಳ ಅನುದಾನದೊಂದಿಗೆ ಈ ಕಾಮಗಾರಿಯನ್ನು ಕೈಗೊಳ್ಳಲು ಅವಕಾಶ ಕಲ್ಪಿಸಿದೆ.

ಮೇಲ್ಕಂಡ ಪ್ರಸ್ತಾವನೆಯನ್ನು ಪರಿಶೀಲಿಸಿ ಸರ್ಕಾರವು ಕೆಳಕಂಡಂತೆ ಆದೇಶಿಸಿದೆ.

**ಸರ್ಕಾರದ ಆದೇಶ ಸಂಖ್ಯೆ : ಸನೀಇ 133 ಅಪಿಬಂ 2012 (ತಾಂತ್ರಿಕ), ಬೆಂಗಳೂರು, ದಿನಾಂಕ : 17ನೇ ಜನವರಿ, 2013.**

ಮೇಲೆ ಪ್ರಸ್ತಾವನೆಯಲ್ಲಿ ವಿವರಿಸಿರುವ ಅಂಶಗಳ ಹಿನ್ನೆಲೆಯಲ್ಲಿ ಬಾಗಲಕೋಟೆ ಜಿಲ್ಲೆ ಹುನಗುಂದ ತಾಲ್ಲೂಕು ಹುನಗುಂದ ಪಟ್ಟಣದ ಹತ್ತಿರ ಹಿರೇಹಳ್ಳಕ್ಕೆ ಬ್ರಿಡ್ಜ್ ಕಂ ಬ್ಯಾರೇಜ್ ನಿರ್ಮಾಣ ಕಾಮಗಾರಿಯ ರೂ. 297.50 ಲಕ್ಷ ಮೊತ್ತದ ಅಂದಾಜಿಗೆ (ರೂ. ಎರಡು ಕೋಟಿ ತೊಂಬತ್ತೇಳು ಲಕ್ಷ ಐವತ್ತು ಸಾವಿರ ಮಾತ್ರ) ಮೊತ್ತದ ಅಂದಾಜು ಪಟ್ಟಿಗೆ ಸರ್ಕಾರವು ಈ ಕೆಳಕಂಡ ಷರತ್ತುಗಳಿಗೊಳಪಟ್ಟು ಆಡಳಿತಾತ್ಮಕ ಅನುಮೋದನೆ ನೀಡಿದೆ.

1. ಕಾಮಗಾರಿಯ ಅನುಷ್ಠಾನ ಪೂರ್ವ ಹಾಗೂ ಅನುಷ್ಠಾನ ನಂತರದ ಫಲಶೃತಿಗಳನ್ನು ದಾಖಲಿಸುವುದು.
2. ಕಾಮಗಾರಿಗಳ ವಿವಿಧ ಅನುಷ್ಠಾನ ಹಂತದ ವೀಡಿಯೋ ಹಾಗೂ ಛಾಯಾಚಿತ್ರಗಳನ್ನು ದಾಖಲಿಸುವುದು.
3. ಕಾಮಗಾರಿಯ ವೆಚ್ಚವು ಯಾವುದೇ ಕಾರಣಕ್ಕೂ ಅನುಮೋದಿಸಿದ ಟೆಂಡರ್ ಮೊತ್ತಕ್ಕಿಂತ ಹೆಚ್ಚಾಗಬಾರದು ಹಾಗೂ ಕಾಮಗಾರಿಯನ್ನು ಕಾಲಮಿತಿಯೊಳಗೆ ಪೂರ್ಣಗೊಳಿಸತಕ್ಕದ್ದು.
4. ಒಂದು ವೇಳೆ ಸ್ಥಳ ಪರಿಸ್ಥಿತಿಗೆ ಅನುಗುಣವಾಗಿ ಹೆಚ್ಚಳ ನಿರೀಕ್ಷಿಸಿದಲ್ಲಿ ತಕ್ಷಣವೇ ಸಕ್ಷಮ ಪ್ರಾಧಿಕಾರದಿಂದ ಅನುಮೋದನೆ ಪಡೆದು ಕಾಮಗಾರಿಯನ್ನು ಪೂರ್ಣಗೊಳಿಸತಕ್ಕದ್ದು.
5. ದಿನಾಂಕ : 13–7–2012ರಂದು ನಡೆದ ತಾಂತ್ರಿಕ ಮೌಲ್ಯ ನಿರ್ಣಯ ಸಮಿತಿ ಸಭೆಯಲ್ಲಿ ಸಮಿತಿಯು ಗಮನಿಸಿರುವ ಅಂಶಗಳನ್ನು ಅಳವಡಿಸಿಕೊಳ್ಳುವುದು.
6. ಕಾಮಗಾರಿ ಪ್ರಾರಂಭಿಸುವ ಮುನ್ನ ವಿನ್ಯಾಸ ಬದಲಾವಣೆಯಿಂದಾಗಿ ಅಥವಾ ಬೇರೆ ಕಾರಣದಿಂದ ಅನುಮೋದಿಸಿದ ಅಂದಾಜು ಮೊತ್ತ ಹೆಚ್ಚಾಗುವ ಸಂಭವ ಇದ್ದಲ್ಲಿ, ತಕ್ಷಣ ಪರಿಷ್ಕೃತ ಅಂದಾಜಿಗೆ ಸಕ್ಷಮ ಪ್ರಾಧಿಕಾರದಿಂದ ಅನುಮೋದನೆ ಪಡೆದು ನಂತರ ಕಾಮಗಾರಿಯನ್ನು ಪ್ರಾರಂಭಿಸುವುದು.
7. ಕರ್ನಾಟಕ ಸಾರ್ವಜನಿಕ ಸಂಗ್ರಹಣೆಗಳಲ್ಲಿ ಪಾರದರ್ಶಕತೆ ಅಧಿನಿಯಮ 1999ರ ಅನುಸಾರ ಟೆಂಡರ್ ಕರೆದು ತೆಗೆದುಕೊಳ್ಳತಕ್ಕದ್ದು.
8. ಕಾಮಗಾರಿ ಪೂರ್ಣಗೊಂಡ ಕೂಡಲೇ ಪೂರ್ಣತಾ ವರದಿಯನ್ನು ಸಲ್ಲಿಸತಕ್ಕದ್ದು ಹಾಗೂ ಅವಶ್ಯಕತೆ ಇದ್ದಲ್ಲಿ ಪರಿಷ್ಕೃತ ಅಂದಾಜು ತಯಾರಿಸಿ ಟಿ.ಎ.ಸಿ. ಅನುಮೋದನೆ ಪಡೆದು ಸಂಬಂಧಿಸಿದ ಸಕ್ಷಮ ಅಧಿಕಾರಿಗಳಿಗೆ ಅನುಮೋದನೆಗಾಗಿ ಸಲ್ಲಿಸುವುದು.
9. ಇ.ಐ.ಆರ್.ಎಲ್/ವರ್ಕ್‌ಸ್ಲಿಪ್‌ಗಳನ್ನು ಸಲ್ಲಿಸಬೇಕಾದಲ್ಲಿ ತಕ್ಷಣವೇ ಸಲ್ಲಿಸತಕ್ಕದ್ದು.
10. ತಾಂತ್ರಿಕ ಮಂಜೂರಾತಿಯನ್ನು ನೀಡುವ ಮೊದಲು ಅಂದಾಜನ್ನು ಮೊತ್ತೊಮ್ಮೆ ವಿವರವಾಗಿ ಪರಿಶೀಲಿಸುವುದು.
11. ಈ ಯೋಜನೆಗಳಿಗೆ ನೀರು ಬಳಕೆದಾರರ ಸಂಘವನ್ನು ಸೃಜಿಸಬೇಕು ಹಾಗೂ ನಿರ್ವಹಣೆಯನ್ನು ಸದರಿ ಸಂಘಕ್ಕೆ ವಹಿಸತಕ್ಕದ್ದು.

ಈ ಆದೇಶವನ್ನು ಸರ್ಕಾರದ ಆದೇಶ ಸಂಖ್ಯೆ : ಎಫ್‌ಡಿ 1 ಟಿಎಫ್‌ಪಿ 2008, ದಿನಾಂಕ : 16–5–2008ರಲ್ಲಿ ಇಲಾಖಾ ಕಾರ್ಯದರ್ಶಿಯವರಿಗೆ ನೀಡಲಾದ ಆರ್ಥಿಕ ಅಧಿಕಾರದನ್ವಯ ಹೊರಡಿಸಲಾಗಿದೆ.

ಕರ್ನಾಟಕ ರಾಜ್ಯಪಾಲರ ಆದೇಶಾನುಸಾರ ಮತ್ತು ಅವರ ಹೆಸರಿನಲ್ಲಿ

**ರುದ್ರಮೂರ್ತಿ**

ಪದನಿಮಿತ್ತ ಸರ್ಕಾರದ ಅಧೀನ ಕಾರ್ಯದರ್ಶಿ,

P.R. 119

ಜಲಸಂಪನ್ಮೂಲ ಇಲಾಖೆ (ಸಣ್ಣ ನೀರಾವರಿ).

## ಜಲಸಂಪನ್ಮೂಲ ಸಚಿವಾಲಯ

**ವಿಷಯ :** ಬಾಗಲಕೋಟೆ ಜಿಲ್ಲೆ ಹಾಗೂ ತಾಲ್ಲೂಕು ಖಜ್ಜಿಡೋಣಿ–ಉದಗಟ್ಟಿ ಹತ್ತಿರ ಹಳ್ಳಕ್ಕೆ ಬ್ರಿಡ್ಜ್ ಕಂ ಬ್ಯಾರೇಜ್ ನಿರ್ಮಾಣ ಕಾಮಗಾರಿಯ ಅಂದಾಜಿಗೆ ಆಡಳಿತಾತ್ಮಕ ಅನುಮೋದನೆ ನೀಡುವ ಬಗ್ಗೆ.

**ಓದಲಾಗಿದೆ :** ಮುಖ್ಯ ಇಂಜಿನಿಯರ್, ಸಣ್ಣ ನೀರಾವರಿ ಉತ್ತರ ವಲಯ ಬಿಜಾಪುರರವರ ಪತ್ರದ ಸಂಖ್ಯೆ: ಮುಇಂ/ಸನೀ(ಉ)ವಲಯ/ಬಿಜೆಪಿ/ಎಇ–6/2011–12/4628, ದಿನಾಂಕ : 14–8–2012

**ಪ್ರಸ್ತಾವನೆ :**

ಬಾಗಲಕೋಟೆ ಜಿಲ್ಲೆ ಹಾಗೂ ತಾಲ್ಲೂಕು ಖಜ್ಜಿಡೋಣಿ–ಉದಗಟ್ಟಿ ಹತ್ತಿರ ಹಳ್ಳಕ್ಕೆ ಬ್ರಿಡ್ಜ್ ಕಂ ಬ್ಯಾರೇಜ್ ನಿರ್ಮಾಣ ಕಾಮಗಾರಿಯ 2012–13ನೇ ಸಾಲಿಗೆ ಮುಂದುವರೆಸಲಾದ 2010–11ನೇ ಸಾಲಿನ ದರಪಟ್ಟಿಯ ದರಗಳನ್ನಳವಡಿಸಿ ಸಿದ್ದಪಡಿಸಿರುವ ರೂ. 230.00 ಲಕ್ಷ ಅಂದಾಜು ಪಟ್ಟಿಗೆ ಆಡಳಿತಾತ್ಮಕ ಅನುಮೋದನೆ ಕೋರಿ ಮೇಲೆ ಓದಲಾದ ಪತ್ರದೊಂದಿಗೆ ಮುಖ್ಯ ಇಂಜಿನಿಯರ್, ಸಣ್ಣ ನೀರಾವರಿ ಉತ್ತರ ವಲಯ ಬಿಜಾಪುರರವರು ಪ್ರಸ್ತಾವನೆ ಸಲ್ಲಿಸಿರುತ್ತಾರೆ.

ಉದ್ದೇಶಿತ ಬ್ಯಾರೇಜಿನ ಉದ್ದ–94.00ಮೀ ಮೇಲ್ಭಾಗದಲ್ಲಿ 6.00 ಮೀ ಅಗಲ, ಮತ್ತು ಎತ್ತರ 2.00 ಮೀಗಳಾಗಿದ್ದು 18 ಮುಖ್ಯ ನಡುಗಂಬಗಳು ಹಾಗೂ 19 ನೆಪಮಾತ್ರ ನಡುಗಂಬಗಳು ಮತ್ತು 38 ಕಿಂಡಿಗಳೊಂದಿಗೆ ನಿರ್ಮಿಸಲು ವಿನ್ಯಾಸಿಸಲಾಗಿರುತ್ತದೆ. ನೀರಿನ ಶೇಖರಣಾ ಸಾಮರ್ಥ್ಯವು 10.53 ದಶಲಕ್ಷ ಘನ ಅಡಿಗಳಾಗಿದ್ದು ಈ ಯೋಜನೆಯ ನಿರ್ಮಾಣದಿಂದ 100 ಹೆಕ್ಟೇರ್ ಪ್ರದೇಶಕ್ಕೆ ನೀರಾವರಿ ಸೌಲಭ್ಯ ಕಲ್ಪಿಸಲು ಉದ್ದೇಶಿಸಲಾಗಿದೆ. ಈ ಯೋಜನೆಯ ಲಾಭ ವೆಚ್ಚದ ಅನುಪಾತ ಶೇಕಡಾ 10ರ ದರದಲ್ಲಿ 1.75 ಆಗಿದ್ದು ಆರ್ಥಿಕವಾಗಿ ಶಕ್ಯವಾಗಿರುತ್ತದೆ.

ಈ ಕಾಮಗಾರಿಯ ಅಂದಾಜನ್ನು ದಿನಾಂಕ : 13–7–2012ರಂದು ನಡೆದ ತಾಂತ್ರಿಕ ಮೌಲ್ಯ ನಿರ್ಣಯ ಸಮಿತಿ ಸಭೆಯ ಮುಂದೆ ಮಂಡಿಸಲಾಗಿದ್ದು ಸಮಿತಿಯು ಕೆಲವು ಷರಾಗಳೊಂದಿಗೆ ತೀರುವಳಿ ನೀಡಿರುತ್ತದೆ.

2012–13ನೇ ಸಾಲಿನ ಅಪೆಂಡಿಕ್ಸ್–ಇ ಲೆಕ್ಕ ಶೀರ್ಷಿಕೆ "4702–00–101–5–01–139 ಅಣೆಕಟ್ಟು ಮತ್ತು ಪಿಕಪ್–ಪ್ರಧಾನ ಕಾಮಗಾರಿಗಳು" ರಡಿಯಲ್ಲಿ ರೂ. 350.00 ಲಕ್ಷ ಅಂದಾಜು ಮೊತ್ತ ಹಾಗೂ ರೂ. 167.67 ಲಕ್ಷಗಳ ಅನುದಾನದೊಂದಿಗೆ ಈ ಕಾಮಗಾರಿಯನ್ನು ಕೈಗೊಳ್ಳಲು ಅವಕಾಶ ಕಲ್ಪಿಸಿದೆ.

ಮೇಲ್ಕಂಡ ಪ್ರಸ್ತಾವನೆಯನ್ನು ಪರಿಶೀಲಿಸಿ ಸರ್ಕಾರವು ಕೆಳಕಂಡಂತೆ ಆದೇಶಿಸಿದೆ.

**ಸರ್ಕಾರದ ಆದೇಶ ಸಂಖ್ಯೆ : ಸನೀಇ 134 ಅಪಿಬಂ 2012 (ತಾಂತ್ರಿಕ), ಬೆಂಗಳೂರು, ದಿನಾಂಕ : 17ನೇ ಜನವರಿ, 2013.**

ಮೇಲೆ ಪ್ರಸ್ತಾವನೆಯಲ್ಲಿ ವಿವರಿಸಿರುವ ಅಂಶಗಳ ಹಿನ್ನೆಲೆಯಲ್ಲಿ ಬಾಗಲಕೋಟೆ ಜಿಲ್ಲೆ ಹಾಗೂ ತಾಲ್ಲೂಕು ಖಜ್ಜಿಡೋಣಿ–ಉದಗಟ್ಟಿ ಹತ್ತಿರ ಹಳ್ಳಕ್ಕೆ ಬ್ರಿಡ್ಜ್ ಕಂ ಬ್ಯಾರೇಜ್ ನಿರ್ಮಾಣ ಕಾಮಗಾರಿಯ ರೂ. 230.00 ಲಕ್ಷ ಮೊತ್ತದ ಅಂದಾಜಿಗೆ (ರೂ. ಎರಡು ಕೋಟಿ ಮೂವತ್ತು ಲಕ್ಷ ಮಾತ್ರ) ಮೊತ್ತದ ಅಂದಾಜು ಪಟ್ಟಿಗೆ ಸರ್ಕಾರವು ಈ ಕೆಳಕಂಡ ಷರತ್ತುಗಳಿಗೊಳಪಟ್ಟು ಆಡಳಿತಾತ್ಮಕ ಅನುಮೋದನೆ ನೀಡಿದೆ.

1. ಕಾಮಗಾರಿಯ ಅನುಷ್ಠಾನ ಪೂರ್ವ ಹಾಗೂ ಅನುಷ್ಠಾನ ನಂತರದ ಫಲಶೃತಿಗಳನ್ನು ದಾಖಲಿಸುವುದು.
2. ಕಾಮಗಾರಿಗಳ ವಿವಿಧ ಅನುಷ್ಠಾನ ಹಂತದ ವೀಡಿಯೋ ಹಾಗೂ ಛಾಯಾಚಿತ್ರಗಳನ್ನು ದಾಖಲಿಸುವುದು.
3. ಕಾಮಗಾರಿಯ ವೆಚ್ಚವು ಯಾವುದೇ ಕಾರಣಕ್ಕೂ ಅನುಮೋದಿಸಿದ ಟೆಂಡರ್ ಮೊತ್ತಕ್ಕಿಂತ ಹೆಚ್ಚಾಗಬಾರದು ಹಾಗೂ ಕಾಮಗಾರಿಯನ್ನು ಕಾಲಮಿತಿಯೊಳಗೆ ಪೂರ್ಣಗೊಳಿಸತಕ್ಕದ್ದು.
4. ಒಂದು ವೇಳೆ ಸ್ಥಳ ಪರಿಸ್ಥಿತಿಗೆ ಅನುಗುಣವಾಗಿ ಹೆಚ್ಚಳ ನಿರೀಕ್ಷಿಸಿದಲ್ಲಿ ತಕ್ಷಣವೇ ಸಕ್ಷಮ ಪ್ರಾಧಿಕಾರದಿಂದ ಅನುಮೋದನೆ ಪಡೆದು ಕಾಮಗಾರಿಯನ್ನು ಪೂರ್ಣಗೊಳಿಸತಕ್ಕದ್ದು.
5. ದಿನಾಂಕ : 13–7–2012ರಂದು ನಡೆದ ತಾಂತ್ರಿಕ ಮೌಲ್ಯ ನಿರ್ಣಯ ಸಮಿತಿ ಸಭೆಯಲ್ಲಿ ಸಮಿತಿಯು ಗಮನಿಸಿರುವ ಅಂಶಗಳನ್ನು ಅಳವಡಿಸಿಕೊಳ್ಳುವುದು.
6. ಕಾಮಗಾರಿ ಪ್ರಾರಂಭಿಸುವ ಮುನ್ನ ವಿನ್ಯಾಸ ಬದಲಾವಣೆಯಿಂದಾಗಿ ಅಥವಾ ಬೇರೆ ಕಾರಣದಿಂದ ಅನುಮೋದಿಸಿದ ಅಂದಾಜು ಮೊತ್ತ ಹೆಚ್ಚಾಗುವ ಸಂಭವ ಇದ್ದಲ್ಲಿ, ತಕ್ಷಣ ಪರಿಷ್ಕೃತ ಅಂದಾಜಿಗೆ ಸಕ್ಷಮ ಪ್ರಾಧಿಕಾರದಿಂದ ಅನುಮೋದನೆ ಪಡೆದು ನಂತರ ಕಾಮಗಾರಿಯನ್ನು ಪ್ರಾರಂಭಿಸುವುದು.
7. ಕರ್ನಾಟಕ ಸಾರ್ವಜನಿಕ ಸಂಗ್ರಹಣೆಗಳಲ್ಲಿ ಪಾರದರ್ಶಕತೆ ಅಧಿನಿಯಮ 1999ರ ಅನುಸಾರ ಟೆಂಡರ್ ಕರೆದು ತೆಗೆದುಕೊಳ್ಳತಕ್ಕದ್ದು.
8. ಕಾಮಗಾರಿ ಪೂರ್ಣಗೊಂಡ ಕೂಡಲೇ ಪೂರ್ಣತಾ ವರದಿಯನ್ನು ಸಲ್ಲಿಸತಕ್ಕದ್ದು ಹಾಗೂ ಅವಶ್ಯಕತೆ ಇದ್ದಲ್ಲಿ ಪರಿಷ್ಕೃತ ಅಂದಾಜು ತಯಾರಿಸಿ ಟಿ.ಎ.ಸಿ. ಅನುಮೋದನೆ ಪಡೆದು ಸಂಬಂಧಿಸಿದ ಸಕ್ಷಮ ಅಧಿಕಾರಿಗಳಿಗೆ ಅನುಮೋದನೆಗಾಗಿ ಸಲ್ಲಿಸುವುದು.
9. ಇ.ಐ.ಆರ್.ಎಲ್/ವರ್ಕ್‌ಸ್ಲಿಪ್‌ಗಳನ್ನು ಸಲ್ಲಿಸಬೇಕಾದಲ್ಲಿ ತಕ್ಷಣವೇ ಸಲ್ಲಿಸತಕ್ಕದ್ದು.

10. ತಾಂತ್ರಿಕ ಮಂಜೂರಾತಿಯನ್ನು ನೀಡುವ ಮೊದಲು ಅಂದಾಜನ್ನು ಮೊತ್ತೊಮ್ಮೆ ವಿವರವಾಗಿ ಪರಿಶೀಲಿಸುವುದು.
11. ಈ ಯೋಜನೆಗಳಿಗೆ ನೀರು ಬಳಕೆದಾರರ ಸಂಘವನ್ನು ಸೃಜಿಸಬೇಕು ಹಾಗೂ ನಿರ್ವಹಣೆಯನ್ನು ಸದರಿ ಸಂಘಕ್ಕೆ ವಹಿಸತಕ್ಕದ್ದು.

ಈ ಆದೇಶವನ್ನು ಸರ್ಕಾರದ ಆದೇಶ ಸಂಖ್ಯೆ : ಎಫ್‌ಡಿ 1 ಟಿಎಫ್‌ಪಿ 2008, ದಿನಾಂಕ : 16-5-2008 ರಲ್ಲಿ ಇಲಾಖಾ ಕಾರ್ಯದರ್ಶಿಯವರಿಗೆ ನೀಡಲಾದ ಆರ್ಥಿಕ ಅಧಿಕಾರದನ್ವಯ ಹೊರಡಿಸಲಾಗಿದೆ.

ಕರ್ನಾಟಕ ರಾಜ್ಯಪಾಲರ ಆದೇಶಾನುಸಾರ ಮತ್ತು ಅವರ ಹೆಸರಿನಲ್ಲಿ
**ರುದ್ರಮೂರ್ತಿ**
ಪದನಿಮಿತ್ತ ಸರ್ಕಾರದ ಅಧೀನ ಕಾರ್ಯದರ್ಶಿ,
ಜಲಸಂಪನ್ಮೂಲ ಇಲಾಖೆ (ಸಣ್ಣ ನೀರಾವರಿ).

P.R. 120

## ಜಲಸಂಪನ್ಮೂಲ ಸಚಿವಾಲಯ

**ವಿಷಯ :** ತುಮಕೂರು ಜಿಲ್ಲೆ, ಪಾವಗಡ ತಾಲ್ಲೂಕು, ದೇವರಬೆಟ್ಟ ಸ.ನಂ. 13 ರಲ್ಲಿ ಚೆಕ್‌ಡ್ಯಾಂ ನಿರ್ಮಾಣ ಕಾಮಗಾರಿಗಳ ಟೆಂಡರ್ ಅನುಮೋದನೆ ಬಗ್ಗೆ.

**ಓದಲಾಗಿದೆ :** ಮುಖ್ಯ ಇಂಜಿನಿಯರ್, ಸಣ್ಣ ನೀರಾವರಿ ದಕ್ಷಿಣ ವಲಯ ಬೆಂಗಳೂರುರವರ ಪತ್ರದ ಸಂಖ್ಯೆ : ಮುಸದ/ತಾಂಸ-1/ಸ.ಇಂ-1/ತುಮಕೂರು/ಟೆಂಡರ್/2012-13/4347, ದಿನಾಂಕ : 15-12-2012.

**ಪ್ರಸ್ತಾವನೆ :**

ತುಮಕೂರು ಜಿಲ್ಲೆ, ಪಾವಗಡ ತಾಲ್ಲೂಕು, ದೇವರಬೆಟ್ಟ ಸ.ನಂ. 13 ರಲ್ಲಿ ಚೆಕ್‌ಡ್ಯಾಂ ನಿರ್ಮಾಣ ಕಾಮಗಾರಿಯ ರೂ. 10.00 ಲಕ್ಷಗಳ ಅಂದಾಜು ಪಟ್ಟಿಗೆ ಕಾರ್ಯಪಾಲಕ ಇಂಜಿನಿಯರ್, ಸಣ್ಣ ನೀರಾವರಿ ವಲಯ, ತುಮಕೂರು ಇವರು ಮಂಜೂರಾತಿ ನೀಡಿರುತ್ತಾರೆ.

ಈ ಕಾಮಗಾರಿಯನ್ನು ಕೈಗೊಳ್ಳಲು ತುಮಕೂರು ಸಣ್ಣ ನೀರಾವರಿ ವಿಭಾಗದಿಂದ ಕರೆಯಲಾದ ಟೆಂಡರ್ ಪ್ರಕಟಣೆಯನ್ನು ಕೆಳಕಂಡ ಮಾಧ್ಯಮಗಳಲ್ಲಿ ಪ್ರಕಟಿಸಲಾಗಿದೆ.

| | ಮೂಲ ಪ್ರಕಟಣೆ | ತಿದ್ದುಪಡಿ ಪ್ರಕಟಣೆ |
|---|---|---|
| ತುಮಕೂರು ಜಿಲ್ಲಾ ಟೆಂಡರ್ ಬುಲೆಟಿನ್ | 27-7-2012 | |
| ಪ್ರಜಾ ಪ್ರಗತಿ ದಿನ ಪತ್ರಿಕೆ | 29-7-2012 | 1-8-2012 |

ದಿನಾಂಕ 13-8-2012ರಂದು ಇ-ಪ್ರೊಕ್ಯೂರ್‌ಮೆಂಟ್ ಮೂಲಕ ಟೆಂಡರ್ ಅನ್ನು ತೆರೆಯಲಾಗಿದ್ದು, ಈ ಟೆಂಡರ್ ಪ್ರಕಟಣೆಗೆ ಸ್ಪಂದಿಸಿ ನಾಲ್ಕು ಜನ ಗುತ್ತಿಗೆದಾರರು ಭಾಗವಹಿಸಿದ್ದು ಇವರಲ್ಲಿ ಒಬ್ಬರ ಟೆಂಡರ್ ಮಾತ್ರ ಅರ್ಹತೆ ಹೊಂದಿದ್ದು, ವಿವರಗಳು ಕೆಳಕಂಡಂತಿವೆ.

| ಮಂಜೂರಾದ ಅಂದಾಜಿನ ದರಗಳಂತೆ ಹಾಗೂ ಪ್ರಸಕ್ತ ಸಾಲಿನ ದರಗಳಿಗೆ ಪರಿಷ್ಕರಿಸಿದಂತೆ ಟೆಂಡರಿಗೆ ಇಡಲಾದ ಮೊತ್ತ | | | ರೂ. 9,99,259/- |
|---|---|---|---|
| ಕ್ರಮ ಸಂಖ್ಯೆ | ಗುತ್ತಿಗೆದಾರರ ಹೆಸರು ಮತ್ತು ದರ್ಜೆ ಶ್ರೀ/ಮೆಸರ್ಸ್ | ಟೆಂಡರ್‌ನಲ್ಲಿ ಗುತ್ತಿಗೆದಾರರು ನಮೂದಿಸಿರುವ ದರಗಳಂತೆ ಟೆಂಡರಿನ ಮೊತ್ತ | ಮಂಜೂರಾದ ಅಂದಾಜಿನ ದರಗಳ ಹಾಗೂ ಪ್ರಸಕ್ತ ಸಾಲಿನ ದರಗಳ ಮೇಲಿನ ಶೇಕಡಾವಾರು ಹೆಚ್ಚಳ/ಕಡಿಮೆ |
| 1. | ಯು. ಹನುಮಂತರಾಯ, 3ನೇ ದರ್ಜೆ ಗುತ್ತಿಗೆದಾರರು | 10,67,740/- | 6.85 ಹೆಚ್ಚು |

ಮೇಲ್ಕಂಡಂತೆ ಶ್ರೀ ಯು. ಹನುಮಂತರಾಯ, 3ನೇ ದರ್ಜೆ ಗುತ್ತಿಗೆದಾರರು ಇವರು ಟೆಂಡರ್‌ನಲ್ಲಿ ಅರ್ಹತೆ ಹೊಂದಿದ ಗುತ್ತಿಗೆದಾರರಾಗಿದ್ದು ಇವರು ನಮೂದಿಸಿದ ದರಗಳನ್ನು ಪ್ರಸಕ್ತ ಸಾಲಿನ ದರಗಳಿಗೆ ಪರಿಷ್ಕರಿಸಿದ ಟೆಂಡರ್‌ಗಿಟ್ಟ ಮೊತ್ತಕ್ಕೆ ಹೋಲಿಸಿದಾಗ ಶೇಕಡ 6.85 ರಷ್ಟು ಹೆಚ್ಚಾಗಿರುತ್ತದೆ. ಸದರಿ ಟೆಂಡರನ್ನು ಸರ್ಕಾರದಲ್ಲಿ ಪರಿಶೀಲಿಸಿ ಪರಿಷ್ಕೃತ ದರಗಳ ಮೇಲೆ ಶೇ. 6.75ರಷ್ಟು ಹೆಚ್ಚಿನ ದರಗಳಿಗೆ ಅಂದರೆ ರೂ. 10,66,709/- ಗಳಿಗೆ ಟೆಂಡರನ್ನು ಅನುಮೋದಿಸಲು ಪರಿಗಣಿಸಿದೆ.

ಮೇಲಿನ ಅಂಶಗಳ ಹಿನ್ನಲೆಯಲ್ಲಿ ಸರ್ಕಾರವು ಈ ಕೆಳಕಂಡಂತೆ ಆದೇಶ ಹೊರಡಿಸಿದೆ.

**ಸರ್ಕಾರದ ಆದೇಶ ಸಂಖ್ಯೆ : ಸನೀಇ 136 ಅಪಿಬಂ 2012 (ತಾಂತ್ರಿಕ), ಬೆಂಗಳೂರು, ದಿನಾಂಕ : 15ನೇ ಜನವರಿ, 2013.**

ಪ್ರಸ್ತಾವನೆಯಲ್ಲಿ ವಿವರಿಸಿರುವ ಅಂಶಗಳ ಹಿನ್ನೆಲೆಯಲ್ಲಿ ತುಮಕೂರು ಜಿಲ್ಲೆ, ಪಾವಗಡ ತಾಲ್ಲೂಕು, ದೇವರಬೆಟ್ಟ ಸ.ನಂ. 13 ರಲ್ಲಿ ಚೆಕ್‌ಡ್ಯಾಂ ನಿರ್ಮಾಣ ಕಾಮಗಾರಿಯನ್ನು ಪ್ರಸಕ್ತ ಸಾಲಿನ ದರಪಟ್ಟಿಯ ದರಗಳನ್ನು ಪರಿಗಣಿಸಿ ಪರಿಷ್ಕರಿಸಿದಂತೆ ಟೆಂಡರಿಗಿಟ್ಟ ಮೊತ್ತ ರೂ. 9,99,259/-ಗಳ ಮೇಲೆ ಶೇ. 6.75ರಷ್ಟು ಹೆಚ್ಚಿನ ದರದಲ್ಲಿ ಅಂದರೆ ರೂ. 10,66,709/-ಗಳಿಗೆ (ರೂ. ಹತ್ತು ಲಕ್ಷ ಅರವತ್ತ ಆರು ಸಾವಿರದ ಏಳು ನೂರ ಒಂಬತ್ತು ರೂಪಾಯಿಗಳು ಮಾತ್ರ) ಶ್ರೀ ಯು. ಹನುಮಂತರಾಯ, 3ನೇ ದರ್ಜೆ ಗುತ್ತಿಗೆದಾರರಿಗೆ ಕೆಳಕಂಡ ಷರತ್ತುಗಳಿಗೆ ಒಳಪಡಿಸಿ ವಹಿಸಲು ಸರ್ಕಾರವು ಅನುಮೋದನೆ ನೀಡಿದೆ.

1. ಕಾಮಗಾರಿಯನ್ನು ನಿಗದಿತ ಅವಧಿಯಲ್ಲಿ ಪೂರ್ಣಗೊಳಿಸತಕ್ಕದ್ದು.
2. ಸರ್ಕಾರದ ಅನುಮತಿ ಪಡೆಯದೆ ಕಾಮಗಾರಿಯಲ್ಲಿ ಯಾವುದೇ ಹೆಚ್ಚುವರಿ ಕೆಲಸ ನಿರ್ವಹಿಸಬಾರದು.

ಈ ಆದೇಶವನ್ನು ಆರ್ಥಿಕ ಇಲಾಖೆಯ ಆದೇಶ ಸಂಖ್ಯೆ : ಎಫ್‌ಡಿ 1 ಟಿಎಫ್‌ಪಿ 2002, ದಿನಾಂಕ : 20–1–2003 ರಲ್ಲಿ ಇಲಾಖಾ ಕಾರ್ಯದರ್ಶಿಯವರಿಗೆ ನೀಡಿರುವ ಆರ್ಥಿಕಾಧಿಕಾರದನ್ವಯ ಹೊರಡಿಸಲಾಗಿದೆ.

ಕರ್ನಾಟಕ ರಾಜ್ಯಪಾಲರ ಆದೇಶಾನುಸಾರ ಮತ್ತು ಅವರ ಹೆಸರಿನಲ್ಲಿ
**ರುದ್ರಮೂರ್ತಿ**
ಪದನಿಮಿತ್ತ ಸರ್ಕಾರದ ಅಧೀನ ಕಾರ್ಯದರ್ಶಿ,
ಜಲಸಂಪನ್ಮೂಲ ಇಲಾಖೆ (ಸಣ್ಣ ನೀರಾವರಿ).

**P.R. 123**

## ಜಲಸಂಪನ್ಮೂಲ ಸಚಿವಾಲಯ

**ವಿಷಯ** : ಧಾರವಾಡ ಜಿಲ್ಲೆ ಕುಂದಗೋಳ ತಾಲ್ಲೂಕಿನ ಹೊಸಳ್ಳಿ ಗ್ರಾಮದ ಹತ್ತಿರ ಗೋಗಿ ಹಳ್ಳಕ್ಕೆ ಅಡ್ಡಲಾಗಿ ಬ್ಯಾರೇಜ್ ನಿರ್ಮಾಣ ಕಾಮಗಾರಿಯ ಟೆಂಡರ್ ಅನುಮೋದಿಸುವ ಬಗ್ಗೆ.

**ಓದಲಾಗಿದೆ :**
1. ಸರ್ಕಾರದ ಆದೇಶ ಸಂಖ್ಯೆ : ಸನೀಇ 12 ಮಸಾವಿ 2011 (18) ತಾಂತ್ರಿಕ, ದಿನಾಂಕ : 11–8–2011.
2. ಮುಖ್ಯ ಇಂಜಿನಿಯರ್, ಸಣ್ಣ ನೀರಾವರಿ ಉತ್ತರ ವಲಯ ಬಿಜಾಪುರರವರ ಪತ್ರದ ಸಂಖ್ಯೆ: ಮುಇಂ/ಸನೀ(ಉ)ವಲಯ/ಬಿಜೆಪಿ/ಎಇ–3/2012–13/6552, ದಿನಾಂಕ : 5–12–2012

**ಪ್ರಸ್ತಾವನೆ :**

ಎ.ಐ.ಬಿ.ಪಿ. ಕಾರ್ಯಕ್ರಮದಡಿ ಧಾರವಾಡ ಜಿಲ್ಲೆ ಕುಂದಗೋಳ ತಾಲ್ಲೂಕಿನ ಹೊಸಳ್ಳಿ ಗ್ರಾಮದ ಹತ್ತಿರ ಗೋಗಿ ಹಳ್ಳಕ್ಕೆ ಅಡ್ಡಲಾಗಿ ಬ್ಯಾರೇಜ್ ನಿರ್ಮಾಣ ಕಾಮಗಾರಿ ಅಂದಾಜಿಗೆ ಉಲ್ಲೇಖ (1) ರಲ್ಲಿ ನಮೂದಿಸಿರುವ ಸರ್ಕಾರದ ಆದೇಶದಲ್ಲಿ ರೂ. 170.00 ಲಕ್ಷಗಳಿಗೆ ಆಡಳಿತಾತ್ಮಕ ಅನುಮೋದನೆ ನೀಡಲಾಗಿದ್ದು ಮುಖ್ಯ ಇಂಜಿನಿಯರ್, ಸಣ್ಣ ನೀರಾವರಿ ಉತ್ತರ ವಲಯ ಬಿಜಾಪುರರವರು ತಾಂತ್ರಿಕ ಮಂಜೂರಾತಿ ನೀಡಿರುತ್ತಾರೆ. ಈ ಕಾಮಗಾರಿಯನ್ನು ಕೈಗೊಳ್ಳಲು ಭಾರತ ಸರ್ಕಾರದ ಅನುಮೋದನೆ ದೊರಕಿರುತ್ತದೆ.

ಈ ಕಾಮಗಾರಿಯನ್ನು ಕೈಗೊಳ್ಳಲು ಧಾರವಾಡ ಸಣ್ಣ ನೀರಾವರಿ ವಿಭಾಗದಿಂದ ಕರ್ನಾಟಕ ಸಾರ್ವಜನಿಕ ಸಂಗ್ರಹಣೆಗಳಲ್ಲಿ ಪಾರದರ್ಶಕತೆ ಅಧಿನಿಯಮದಡಿ ಇ–ಪ್ರೊಕ್ಯೂರ್‌ಮೆಂಟ್ ಮೂಲಕ ಕರೆಯಲಾದ ಟೆಂಡರ್ ಪ್ರಕಟಣೆಯನ್ನು ಕೆಳಕಂಡ ಮಾಧ್ಯಮಗಳಲ್ಲಿ ಪ್ರಕಟಿಸಲಾಗಿದೆ.

| | |
|---|---|
| ರಾಜ್ಯ ಟೆಂಡರ್ ಬುಲೆಟಿನ್ | 28–9–2012 |
| ಜಿಲ್ಲಾ ಟೆಂಡರ್ ಬುಲೆಟಿನ್ | 22–9–2012 |
| ಸಂಯುಕ್ತ ಕರ್ನಾಟಕ ದಿನಪತ್ರಿಕೆ | 29–9–2012 |
| ವಿಜಯ ಕರ್ನಾಟಕ ದಿನ ಪತ್ರಿಕೆ | 28–9–2012 |
| ದಿ ನ್ಯೂ ಇಂಡಿಯನ್ ಎಕ್ಸ್‌ಪ್ರೆಸ್ ಆಂಗ್ಲ ದಿನಪತ್ರಿಕೆ | 28–9–2012 |

ದಿನಾಂಕ : 17–10–2012 ರಂದು ಇ–ಪ್ರೊಕ್ಯೂರ್‌ಮೆಂಟ್ ಮೂಲಕ ಟೆಂಡರ್‌ನ ತಾಂತ್ರಿಕ ಬಿಡ್‌ಅನ್ನು ತೆರೆದು ಪರಿಶೀಲಿಸಲಾಗಿರುತ್ತದೆ. ಈ ಟೆಂಡರ್ ಪ್ರಕಟಣೆಗೆ ಸ್ಪಂದಿಸಿ ಐದು ಜನ ಗುತ್ತಿಗೆದಾರರು ಭಾಗವಹಿಸಿದ್ದು ಈ ಪೈಕಿ ಇಬ್ಬರು ಗುತ್ತಿಗೆದಾರರು ಮಾತ್ರ ಅರ್ಹತೆ ಹೊಂದಿರುತ್ತಾರೆ. ಇವರ ಆರ್ಥಿಕ ಬಿಡ್ ಅನ್ನು ದಿನಾಂಕ : 3–12–2012ರಂದು ತೆರೆಯಲಾಗಿದ್ದು ವಿವರಗಳು ಕೆಳಕಂಡಂತಿವೆ.

| | | | |
|---|---|---|---|
| ಮಂಜೂರಾದ ಅಂದಾಜಿನ ದರಗಳಂತೆ ಟೆಂಡರಿಗೆ ಇಡಲಾದ ಮೊತ್ತ | | | ರೂ. 1,50,71,621/– |
| ಪ್ರಸಕ್ತ ಸಾಲಿನ ದರಗಳನ್ನು ಪರಿಗಣಿಸಿ ಪರಿಷ್ಕರಿಸಿದಂತೆ ಟೆಂಡರಿಗೆ ಇಡಲಾದ ಮೊತ್ತ | | | ರೂ. 1,52,10,613/– |
| ಗುತ್ತಿಗೆದಾರರ ಹೆಸರು ಮತ್ತು ದರ್ಜೆ ಶ್ರೀ/ಮೆಸರ್ಸ್ | ಟೆಂಡರ್‌ನಲ್ಲಿ ಗುತ್ತಿಗೆದಾರರು ನಮೂದಿಸಿರುವ ದರಗಳಂತೆ ಟೆಂಡರಿನ ಮೊತ್ತ | ಮಂಜೂರಾದ ಅಂದಾಜಿನ ದರಗಳ ಮೇಲಿನ ಶೇಕಡಾವಾರು ಹೆಚ್ಚಳ/ಕಡಿಮೆ | ಪರಿಷ್ಕರಿಸಿದ ದರಗಳ ಮೇಲಿನ ಶೇಕಡಾವಾರು ಹೆಚ್ಚಳ/ಕಡಿಮೆ |
| ಅಶೋಕ ಎಸ್. ಶೆಟ್ಟಿ ಒಂದನೇ ದರ್ಜೆ ಗುತ್ತಿಗೆದಾರರು | 1,77,28,333/– | 17.63 ಹೆಚ್ಚು | 16.55 ಹೆಚ್ಚು |
| ಜೆ.ಎನ್. ಶೆಟ್ಟಿ, ಒಂದನೇ ದರ್ಜೆ ಗುತ್ತಿಗೆದಾರರು | 1,90,50,023/– | 26.40 ಹೆಚ್ಚು | 25.24 ಹೆಚ್ಚು |

ಮೇಲ್ಕಂಡಂತೆ ಶ್ರೀ ಅಶೋಕ್ ಎಸ್. ಶೆಟ್ಟಿ, ಒಂದನೇ ದರ್ಜೆ ಗುತ್ತಿಗೆದಾರರು ಇವರು ಟೆಂಡರ್‌ನಲ್ಲಿ ಅರ್ಹತೆ ಹೊಂದಿರುವ ಗುತ್ತಿಗೆದಾರರಾಗಿದ್ದು ಇವರು ನಮೂಸಿದ ದರಗಳನ್ನು ಪ್ರಸಕ್ತ ಸಾಲಿನ ದರಗಳಿಗೆ ಪರಿಷ್ಕರಿಸಿದ ಟೆಂಡರ್‌ಗಿಟ್ಟ ಮೊತ್ತಕ್ಕೆ ಹೋಲಿಸಿದಾಗ ಶೇಕಡ 16.55 ರಷ್ಟು ಹೆಚ್ಚಾಗಿದ್ದು, ಸದರಿಯವರ ಟೆಂಡರನ್ನು ಸಂಧಾನದ ಮೂಲಕ ಅಂಗೀಕರಿಸಲು ಮುಖ್ಯ ಇಂಜಿನಿಯರ್, ಸಣ್ಣ ನೀರಾವರಿ ಉತ್ತರ ವಲಯ, ಬಿಜಾಪುರ ಇವರು ಮೇಲೆ (2) ರಲ್ಲಿ ಓದಲಾದ ಪತ್ರದಲ್ಲಿ ಶಿಫಾರಸ್ಸು ಮಾಡಿರುತ್ತಾರೆ.

ಈ ಟೆಂಡರನ್ನು ಸರ್ಕಾರದಲ್ಲಿ ಪರಿಶೀಲಿಸಿ ಪ್ರಸಕ್ತ ಸಾಲಿನ ದರಗಳಿಗೆ ಪರಿಷ್ಕರಿಸಿದಂತೆ ಟೆಂಡರಿಗಿಟ್ಟ ಪರಿಷ್ಕೃತ ಮೊತ್ತ ರೂ. 1,52,10,613/– ಗಳ ಮೇಲೆ ಶೇಕಡಾ 14.00 ರಷ್ಟು ಹೆಚ್ಚಿನ ದರಗಳಿಗೆ ಅಂದರೆ ರೂ. 1,73,40,099/–ಗಳಿಗೆ ಟೆಂಡರನ್ನು ಅನುಮೋದಿಸಲು ಪರಿಗಣಿಸಿದೆ.

ಮೇಲಿನ ಅಂಶಗಳ ಹಿನ್ನೆಲೆಯಲ್ಲಿ ಸರ್ಕಾರವು ಈ ಕೆಳಕಂಡಂತೆ ಆದೇಶ ಹೊರಡಿಸಿದೆ.

**ಸರ್ಕಾರದ ಆದೇಶ ಸಂಖ್ಯೆ : ಸನೀಇ 135 ಅಪಿಬಂ (ತಾಂತ್ರಿಕ) 2012, ಬೆಂಗಳೂರು, ದಿನಾಂಕ : 3ನೇ ಜನವರಿ, 2012.**

ಪ್ರಸ್ತಾವನೆಯಲ್ಲಿ ವಿವರಿಸಿರುವ ಅಂಶಗಳ ಹಿನ್ನೆಲೆಯಲ್ಲಿ ಧಾರವಾಡ ಜಿಲ್ಲೆ ಕುಂದಗೊಳ ತಾಲ್ಲೂಕಿನ ಹೊಸಳ್ಳಿ ಗ್ರಾಮದ ಹತ್ತಿರ ಗೋಗಿ ಹಳ್ಳಕ್ಕೆ ಅಡ್ಡಲಾಗಿ ಬ್ಯಾರೇಜ್ ನಿರ್ಮಾಣ ಕಾಮಗಾರಿಯನ್ನು ಪ್ರಸಕ್ತ ಸಾಲಿನ ದರಪಟ್ಟಿಯ ದರಗಳನ್ನು ಪರಿಗಣಿಸಿ ಪರಿಷ್ಕರಿಸಿದಂತೆ ಟೆಂಡರಿಗಿಡಲಾದ ಮೊತ್ತ ರೂ. 1,52,10,613/–ಗಳ ಮೇಲೆ ಶೇ. 14.00 ರಷ್ಟು ಹೆಚ್ಚಿನ ದರಗಳಿಗೆ ಅಂದರೆ ರೂ. 1,73,40,099/–ಗಳಿಗೆ (ರೂ. ಒಂದು ಕೋಟಿ ಎಪ್ಪತ್ತಮೂರು ಲಕ್ಷ ನಲವತ್ತು ಸಾವಿರದ ತೊಂಬತ್ತೊಂಬತ್ತು ಮಾತ್ರ) ಗಳಿಗೆ ಶ್ರೀ ಅಶೋಕ ಎಸ್. ಶೆಟ್ಟಿ, ಒಂದನೇ ದರ್ಜೆ ಗುತ್ತಿಗೆದಾರರು ರವರಿಗೆ ಕೆಳಕಂಡ ಷರತ್ತುಗಳಿಗೆ ಒಳಪಡಿಸಿ ವಹಿಸಲು ಸರ್ಕಾರವು ಅನುಮೋದನೆ ನೀಡಿದೆ.

1. ಕಾಮಗಾರಿಯನ್ನು ನಿಗಧಿತ ಅವಧಿಯಲ್ಲಿ ಪೂರ್ಣಗೊಳಿಸತಕ್ಕದ್ದು.
2. ಸರ್ಕಾರದ ಅನುಮತಿ ಪಡೆಯದೆ ಕಾಮಗಾರಿಯಲ್ಲಿ ಯಾವುದೇ ಹೆಚ್ಚುವರಿ ಕೆಲಸ ನಿರ್ವಹಿಸಬಾರದು.

ಈ ಆದೇಶವನ್ನು ಆರ್ಥಿಕ ಇಲಾಖೆಯ ಆದೇಶ ಸಂಖ್ಯೆ : ಎಫ್‌ಡಿ 1 ಟಿಎಫ್‌ಪಿ 2002, ದಿನಾಂಕ : 20–1–2003 ರಲ್ಲಿ ಇಲಾಖಾ ಕಾರ್ಯದರ್ಶಿಯವರಿಗೆ ನೀಡಿರುವ ಆರ್ಥಿಕಾಧಿಕಾರದನ್ವಯ ಹೊರಡಿಸಲಾಗಿದೆ.

ಕರ್ನಾಟಕ ರಾಜ್ಯಪಾಲರ ಆದೇಶಾನುಸಾರ ಮತ್ತು ಅವರ ಹೆಸರಿನಲ್ಲಿ

**ರುದ್ರಮೂರ್ತಿ**

ಪದನಿಮಿತ್ತ ಸರ್ಕಾರದ ಅಧೀನ ಕಾರ್ಯದರ್ಶಿ,

ಜಲಸಂಪನ್ಮೂಲ ಇಲಾಖೆ (ಸಣ್ಣ ನೀರಾವರಿ).

P.R. 101

## ಜಲಸಂಪನ್ಮೂಲ ಸಚಿವಾಲಯ

**ವಿಷಯ :** ಬೆಳಗಾವಿ ಜಿಲ್ಲೆ ಹಾಗೂ ತಾಲ್ಲೂಕಿನ ಹಂದಿಗನೂರ ಗ್ರಾಮದ ಹತ್ತಿರ ಸ್ಥಳೀಯ ನಾಲಾಕ್ಕೆ ಅಡ್ಡಲಾಗಿ ಸೇತುವೆ ಸಹಿತ ಬ್ಯಾರೇಜ್ ನಿರ್ಮಾಣ ಕಾಮಗಾರಿಯ ಟೆಂಡರ್ ಅನುಮೋದಿಸುವ ಬಗ್ಗೆ.

**ಓದಲಾಗಿದೆ :**
1. ಸರ್ಕಾರದ ಆದೇಶ ಸಂಖ್ಯೆ : ಸನೀಇ 12 ಮಸಾವಿ 2011 (17) ತಾಂತ್ರಿಕ, ದಿನಾಂಕ: 11–8–2011.
2. ಮುಖ್ಯ ಇಂಜಿನಿಯರ್, ಸಣ್ಣ ನೀರಾವರಿ ಉತ್ತರ ವಲಯ ಬಿಜಾಪುರರವರ ಪತ್ರದ ಸಂಖ್ಯೆ: ಮುಇಂ/ಸನೀ(ಉ)ವಲಯ/ಬಿಜೆಪಿ/ಎಇ–1/2012–13/5828, ದಿನಾಂಕ : 26–10–2012

**ಪ್ರಸ್ತಾವನೆ :**

ಬೆಳಗಾವಿ ಜಿಲ್ಲೆ ಹಾಗೂ ತಾಲ್ಲೂಕಿನ ಹಂದಿಗನೂರ ಗ್ರಾಮದ ಹತ್ತಿರ ಸ್ಥಳೀಯ ನಾಲಾಕ್ಕೆ ಅಡ್ಡಲಾಗಿ ಸೇತುವೆ ಸಹಿತ ಬ್ಯಾರೇಜ್ ನಿರ್ಮಾಣ ಕಾಮಗಾರಿಯ ಅಂದಾಜಿಗೆ ಎ.ಐ.ಬಿ.ಪಿ. ಕಾರ್ಯಕ್ರಮದಡಿ ಉಲ್ಲೇಖ (1) ರಲ್ಲಿ ನಮೂದಿಸಿರುವ ಸರ್ಕಾರದ ಆದೇಶದಲ್ಲಿ ರೂ. 100.00 ಲಕ್ಷಗಳಿಗೆ ಆಡಳಿತಾತ್ಮಕ ಅನುಮೋದನೆ ನೀಡಲಾಗಿದ್ದು ಮುಖ್ಯ ಇಂಜಿನಿಯರ್, ಸಣ್ಣ ನೀರಾವರಿ ಉತ್ತರ ವಲಯ ಬಿಜಾಪುರರವರು ತಾಂತ್ರಿಕ ಮಂಜೂರಾತಿ ನೀಡಿರುತ್ತಾರೆ. ಈ ಕಾಮಗಾರಿಯನ್ನು ಕೈಗೊಳ್ಳಲು ಭಾರತ ಸರ್ಕಾರದ ಅನುಮೋದನೆ ದೊರಕಿರುತ್ತದೆ.

ಈ ಕಾಮಗಾರಿಯನ್ನು ಕೈಗೊಳ್ಳಲು ಬೆಳಗಾವಿ ಸಣ್ಣ ನೀರಾವರಿ ವಿಭಾಗದಿಂದ ಕರ್ನಾಟಕ ಸಾರ್ವಜನಿಕ ಸಂಗ್ರಹಣೆಗಳಲ್ಲಿ ಪಾರದರ್ಶಕತೆ ಅಧಿನಿಯಮದಡಿ ಇ-ಪ್ರೊಕ್ಯೂರ್‌ಮೆಂಟ್ ಮೂಲಕ ಕರೆಯಲಾದ ಟೆಂಡರ್ ಪ್ರಕಟಣೆಯನ್ನು ಕೆಳಕಂಡ ಮಾಧ್ಯಮಗಳಲ್ಲಿ ಪ್ರಕಟಿಸಲಾಗಿದೆ.

| | |
|---|---|
| ಜಿಲ್ಲಾ ಟೆಂಡರ್ ಬುಲೆಟಿನ್ | 13–8–2012 |

ದಿನಾಂಕ : 17–10–2012 ರಂದು ಇ–ಪ್ರೊಕ್ಯೂರ್‌ಮೆಂಟ್ ಮೂಲಕ ಟೆಂಡರ್‌ನ ತಾಂತ್ರಿಕ ಬಿಡ್‌ಅನ್ನು ತೆರೆದು ಪರಿಶೀಲಿಸಲಾಗಿರುತ್ತದೆ. ಈ ಟೆಂಡರ್ ಪ್ರಕಟಣೆಗೆ ಸ್ಪಂದಿಸಿ ಇಬ್ಬರು ಗುತ್ತಿಗೆದಾರರು ಭಾಗವಹಿಸಿದ್ದು ಇವರು ಅರ್ಹತೆ ಹೊಂದಿರುತ್ತಾರೆ. ಇವರ ಆರ್ಥಿಕ ಬಿಡ್‌ಅನ್ನು ದಿನಾಂಕ : 3–10–2012ರಂದು ತೆರೆಯಲಾಗಿದ್ದು ವಿವರಗಳು ಕೆಳಕಂಡಂತಿವೆ.

| | | | |
|---|---|---|---|
| ಮಂಜೂರಾದ ಅಂದಾಜಿನ ದರಗಳಂತೆ ಟೆಂಡರಿಗೆ ಇಡಲಾದ ಮೊತ್ತ | | | ರೂ. 63,23,312/– |
| ಪ್ರಸಕ್ತ ಸಾಲಿನ ದರಗಳನ್ನು ಪರಿಗಣಿಸಿ ಪರಿಷ್ಕರಿಸಿದಂತೆ ಟೆಂಡರಿಗೆ ಇಡಲಾದ ಮೊತ್ತ | | | ರೂ. 66,41,225/– |
| ಗುತ್ತಿಗೆದಾರರ ಹೆಸರು ಮತ್ತು ದರ್ಜೆ ಶ್ರೀ/ಮೆಸರ್ಸ್ | ಟೆಂಡರ್‌ನಲ್ಲಿ ಗುತ್ತಿಗೆದಾರರು ನಮೂದಿಸಿರುವ ದರಗಳಂತೆ ಟೆಂಡರಿನ ಮೊತ್ತ | ಮಂಜೂರಾದ ಅಂದಾಜಿನ ದರಗಳ ಮೇಲಿನ ಶೇಕಡಾವಾರು ಹೆಚ್ಚಳ/ಕಡಿಮೆ | ಪರಿಷ್ಕರಿಸಿದ ದರಗಳ ಮೇಲಿನ ಶೇಕಡಾವಾರು ಹೆಚ್ಚಳ/ಕಡಿಮೆ |
| ಮೋತಿ ಚಂದ ಎಸ್. ದರಗಶೆಟ್ಟಿ, ಒಂದನೇ ದರ್ಜೆ ಗುತ್ತಿಗೆದಾರರು | 75,78,478/– | 19.85 ಹೆಚ್ಚು | 14.11 ಹೆಚ್ಚು |
| ಪ್ರಕಾಶ ಬಿ. ಬೆಣಚಿನಮರಡಿ. ಒಂದನೇ ದರ್ಜೆ ಗುತ್ತಿಗೆದಾರರು | 75,90,492/– | 20.04 ಹೆಚ್ಚು | 14.29 ಹೆಚ್ಚು |

ಮೇಲ್ಕಂಡಂತೆ ಶ್ರೀ ಮೋತಿಚಂದ ಎಸ್. ದರಗಶೆಟ್ಟಿ, ಒಂದನೇ ದರ್ಜೆ ಗುತ್ತಿಗೆದಾರರು ಇವರು ಟೆಂಡರ್‌ನಲ್ಲಿ ಅರ್ಹತೆ ಹೊಂದಿರುವ ಗುತ್ತಿಗೆದಾರರಾಗಿದ್ದು ಇವರು ನಮೂಸಿದ ದರಗಳನ್ನು ಪ್ರಸಕ್ತ ಸಾಲಿನ ದರಗಳಿಗೆ ಪರಿಷ್ಕರಿಸಿದಂತೆ ಟೆಂಡರ್‌ಗಿಟ್ಟ ಮೊತ್ತಕ್ಕೆ ಹೋಲಿಸಿದಾಗ ಶೇಕಡ 14.11 ರಷ್ಟು ಹೆಚ್ಚಾಗಿದ್ದು, ಸದರಿಯವರ ಟೆಂಡರನ್ನು ಸಂಧಾನದ ಮೂಲಕ ಅಂಗೀಕರಿಸಲು ಮುಖ್ಯ ಇಂಜಿನಿಯರ್, ಸಣ್ಣ ನೀರಾವರಿ ಉತ್ತರ ವಲಯ, ಬಿಜಾಪುರ ಇವರು ಮೇಲೆ (2) ರಲ್ಲಿ ಓದಲಾದ ಪತ್ರದಲ್ಲಿ ಶಿಫಾರಸ್ಸು ಮಾಡಿರುತ್ತಾರೆ.

ಈ ಟೆಂಡರನ್ನು ಸರ್ಕಾರದಲ್ಲಿ ಪರಿಶೀಲಿಸಿ ಪ್ರಸಕ್ತ ಸಾಲಿನ ದರಗಳಿಗೆ ಪರಿಷ್ಕರಿಸಿದಂತೆ ಟೆಂಡರಿಗಿಟ್ಟ ಪರಿಷ್ಕೃತ ಮೊತ್ತ ರೂ. 66,41,225/– ಗಳ ಮೇಲೆ ಶೇಕಡಾ 13.50 ರಷ್ಟು ಹೆಚ್ಚಿನ ದರಗಳಿಗೆ ಅಂದರೆ ರೂ. 75,37,790/–ಗಳಿಗೆ ಟೆಂಡರನ್ನು ಅನುಮೋದಿಸಲು ಪರಿಗಣಿಸಿದೆ.

ಮೇಲಿನ ಅಂಶಗಳ ಹಿನ್ನೆಲೆಯಲ್ಲಿ ಸರ್ಕಾರವು ಈ ಕೆಳಕಂಡಂತೆ ಆದೇಶ ಹೊರಡಿಸಿದೆ.

**ಸರ್ಕಾರದ ಆದೇಶ ಸಂಖ್ಯೆ : ಸನೀಇ 121 ಅಪಿಬಂ (ತಾಂತ್ರಿಕ) 2012, ಬೆಂಗಳೂರು, ದಿನಾಂಕ : 3ನೇ ಜನವರಿ, 2013.**

ಪ್ರಸ್ತಾವನೆಯಲ್ಲಿ ವಿವರಿಸಿರುವ ಅಂಶಗಳ ಹಿನ್ನೆಲೆಯಲ್ಲಿ ಬೆಳಗಾವಿ ಜಿಲ್ಲೆ ಹಾಗೂ ತಾಲ್ಲೂಕಿನ ಹಂದಿಗನೂರ ಗ್ರಾಮದ ಹತ್ತಿರ ಸ್ಥಳೀಯ ನಾಲಾಕ್ಕೆ ಅಡ್ಡಲಾಗಿ ಸೇತುವೆ ಸಹಿತ ಬ್ಯಾರೇಜ್ ನಿರ್ಮಾಣ ಕಾಮಗಾರಿಯನ್ನು ಪ್ರಸಕ್ತ ಸಾಲಿನ ದರಪಟ್ಟಿಯ ದರಗಳನ್ನು ಪರಿಗಣಿಸಿ ಪರಿಷ್ಕರಿಸಿದಂತೆ ಟೆಂಡರಿಗಿಡಲಾದ ಮೊತ್ತ ರೂ. 66,41,225/–ಗಳ ಮೇಲೆ ಶೇ. 13.50 ರಷ್ಟು ಹೆಚ್ಚಿನ ದರಗಳಿಗೆ ಅಂದರೆ ರೂ. 75,37,790/–ಗಳಿಗೆ (ರೂ. ಎಪ್ಪತ್ತೈದು ಲಕ್ಷ ಮೂವತ್ತೇಳು ಸಾವಿರದ ಏಳುನೂರ ತೊಂಬತ್ತು ಮಾತ್ರ) ಗಳಿಗೆ ಶ್ರೀ ಮೋತಿ ಚಂದ ಎಸ್. ದರಗಶೆಟ್ಟಿ, ಒಂದನೇ ದರ್ಜೆ ಗುತ್ತಿಗೆದಾರರು ರವರಿಗೆ ಕೆಳಕಂಡ ಷರತ್ತುಗಳಿಗೆ ಒಳಪಡಿಸಿ ವಹಿಸಲು ಸರ್ಕಾರವು ಅನುಮೋದನೆ ನೀಡಿದೆ.

1. ಕಾಮಗಾರಿಯನ್ನು ನಿಗಧಿತ ಅವಧಿಯಲ್ಲಿ ಪೂರ್ಣಗೊಳಿಸತಕ್ಕದ್ದು.
2. ಸರ್ಕಾರದ ಅನುಮತಿ ಪಡೆಯದೆ ಕಾಮಗಾರಿಯಲ್ಲಿ ಯಾವುದೇ ಹೆಚ್ಚುವರಿ ಕೆಲಸ ನಿರ್ವಹಿಸಬಾರದು.

ಈ ಆದೇಶವನ್ನು ಆರ್ಥಿಕ ಇಲಾಖೆಯ ಆದೇಶ ಸಂಖ್ಯೆ : ಎಫ್‌ಡಿ 1 ಟಿಎಫ್‌ಪಿ 2002, ದಿನಾಂಕ : 20–1–2003 ರಲ್ಲಿ ಇಲಾಖಾ ಕಾರ್ಯದರ್ಶಿಯವರಿಗೆ ನೀಡಿರುವ ಆರ್ಥಿಕಾಧಿಕಾರದನ್ವಯ ಹೊರಡಿಸಲಾಗಿದೆ.

ಕರ್ನಾಟಕ ರಾಜ್ಯಪಾಲರ ಆದೇಶಾನುಸಾರ ಮತ್ತು ಅವರ ಹೆಸರಿನಲ್ಲಿ
**ರುದ್ರಮೂರ್ತಿ**
ಪದನಿಮಿತ್ತ ಸರ್ಕಾರದ ಅಧೀನ ಕಾರ್ಯದರ್ಶಿ,
ಜಲಸಂಪನ್ಮೂಲ ಇಲಾಖೆ (ಸಣ್ಣ ನೀರಾವರಿ).

**P.R. 102**

## ಜಲಸಂಪನ್ಮೂಲ ಸಚಿವಾಲಯ

**ವಿಷಯ :** ಬೆಳಗಾವಿ ಜಿಲ್ಲೆ ಹಾಗೂ ತಾಲ್ಲೂಕಿನ ಕಲ್ಲೆಹೊಳೆ ಗ್ರಾಮದ ಹತ್ತಿರ ಮಾರ್ಕಂಡೇಯ ನದಿಗೆ ಅಡ್ಡಲಾಗಿ ಬ್ಯಾರೇಜ್ ಕಂ ಬ್ರಿಡ್ಜ್ ನಿರ್ಮಾಣ ಕಾಮಗಾರಿಯ ಟೆಂಡರ್ ಅನುಮೋದಿಸುವ ಬಗ್ಗೆ.

**ಓದಲಾಗಿದೆ :**
1. ಸರ್ಕಾರದ ಆದೇಶ ಸಂಖ್ಯೆ : ಸನೀಇ 12 ಮಸಾವಿ 2011 (19) ತಾಂತ್ರಿಕ, ದಿನಾಂಕ: 11–8–2011.
2. ಮುಖ್ಯ ಇಂಜಿನಿಯರ್, ಸಣ್ಣ ನೀರಾವರಿ ಉತ್ತರ ವಲಯ ಬಿಜಾಪುರರವರ ಪತ್ರದ ಸಂಖ್ಯೆ: ಮುಇಂ/ಸನೀ(ಉ)ವಲಯ/ಬಿಜೆಪಿ/ಎಇ–1/2012–13/6138, ದಿನಾಂಕ : 16–11–2012

**ಪ್ರಸ್ತಾವನೆ :**

ಬೆಳಗಾವಿ ಜಿಲ್ಲೆ ಹಾಗೂ ತಾಲ್ಲೂಕಿನ ಕಲ್ಲೆಹೊಳೆ ಗ್ರಾಮದ ಹತ್ತಿರ ಮಾರ್ಕಂಡೇಯ ನದಿಗೆ ಅಡ್ಡಲಾಗಿ ಬ್ಯಾರೇಜ್ ಕಂ ಬ್ರಿಡ್ಜ್ ನಿರ್ಮಾಣ ಕಾಮಗಾರಿ ಅಂದಾಜಿಗೆ ಎ.ಐ.ಬಿ.ಪಿ. ಕಾರ್ಯಕ್ರಮದಡಿ ಉಲ್ಲೇಖ (1) ರಲ್ಲಿ ನಮೂದಿಸಿರುವ ಸರ್ಕಾರದ ಆದೇಶದಲ್ಲಿ ರೂ. 90.00 ಲಕ್ಷಗಳಿಗೆ ಆಡಳಿತಾತ್ಮಕ ಅನುಮೋದನೆ ನೀಡಲಾಗಿದ್ದು ಮುಖ್ಯ ಇಂಜಿನಿಯರ್, ಸಣ್ಣ ನೀರಾವರಿ ಉತ್ತರ ವಲಯ ಬಿಜಾಪುರರವರು ತಾಂತ್ರಿಕ ಮಂಜೂರಾತಿ ನೀಡಿರುತ್ತಾರೆ. ಈ ಕಾಮಗಾರಿಯನ್ನು ಕೈಗೊಳ್ಳಲು ಭಾರತ ಸರ್ಕಾರದ ಅನುಮೋದನೆ ದೊರಕಿರುತ್ತದೆ.

ಈ ಕಾಮಗಾರಿಯನ್ನು ಕೈಗೊಳ್ಳಲು ಬೆಳಗಾವಿ ಸಣ್ಣ ನೀರಾವರಿ ವಿಭಾಗದಿಂದ ಕರ್ನಾಟಕ ಸಾರ್ವಜನಿಕ ಸಂಗ್ರಹಣೆಗಳಲ್ಲಿ ಪಾರದರ್ಶಕತೆ ಅಧಿನಿಯಮದಡಿ ಇ–ಪ್ರೊಕ್ಯೂರ್‌ಮೆಂಟ್ ಮೂಲಕ ಕರೆಯಲಾದ ಟೆಂಡರ್ ಪ್ರಕಟಣೆಯನ್ನು ಕೆಳಕಂಡ ಮಾಧ್ಯಮಗಳಲ್ಲಿ ಪ್ರಕಟಿಸಲಾಗಿದೆ.

| | |
|---|---|
| ಜಿಲ್ಲಾ ಟೆಂಡರ್ ಬುಲೆಟಿನ್ | 13–8–2012 |

ದಿನಾಂಕ : 17–10–2012 ರಂದು ಇ–ಪ್ರೊಕ್ಯೂರ್‌ಮೆಂಟ್ ಮೂಲಕ ಟೆಂಡರ್‌ನ ತಾಂತ್ರಿಕ ಬಿಡ್‌ಅನ್ನು ತೆರೆದು ಪರಿಶೀಲಿಸಲಾಗಿರುತ್ತದೆ. ಈ ಟೆಂಡರ್ ಪ್ರಕಟಣೆಗೆ ಸ್ಪಂದಿಸಿ ಇಬ್ಬರು ಗುತ್ತಿಗೆದಾರರು ಭಾಗವಹಿಸಿದ್ದು ಈ ಪೈಕಿ ಒಬ್ಬರು ಗುತ್ತಿಗೆದಾರರು ಮಾತ್ರ ಅರ್ಹತೆ ಹೊಂದಿರುತ್ತಾರೆ. ಇವರ ಆರ್ಥಿಕ ಬಿಡ್‌ಅನ್ನು ದಿನಾಂಕ : 8–10–2012ರಂದು ತೆರೆಯಲಾಗಿದ್ದು ವಿವರಗಳು ಕೆಳಕಂಡಂತಿವೆ.

| | | | |
|---|---|---|---|
| ಮಂಜೂರಾದ ಅಂದಾಜಿನ ದರಗಳಂತೆ ಟೆಂಡರಿಗೆ ಇಡಲಾದ ಮೊತ್ತ | | | ರೂ. 88,35.295/– |
| ಪ್ರಸಕ್ತ ಸಾಲಿನ ದರಗಳನ್ನು ಪರಿಗಣಿಸಿ ಪರಿಷ್ಕರಿಸಿದಂತೆ ಟೆಂಡರಿಗೆ ಇಡಲಾದ ಮೊತ್ತ | | | ರೂ. 93,01,307/– |
| ಗುತ್ತಿಗೆದಾರರ ಹೆಸರು ಮತ್ತು ದರ್ಜೆ ಶ್ರೀ/ಮೆಸರ್ಸ್ | ಟೆಂಡರ್‌ನಲ್ಲಿ ಗುತ್ತಿಗೆದಾರರು ನಮೂದಿಸಿರುವ ದರಗಳಂತೆ ಟೆಂಡರಿನ ಮೊತ್ತ | ಮಂಜೂರಾದ ಅಂದಾಜಿನ ದರಗಳ ಮೇಲಿನ ಶೇಕಡಾವಾರು ಹೆಚ್ಚಳ/ಕಡಿಮೆ | ಪರಿಷ್ಕರಿಸಿದ ದರಗಳ ಮೇಲಿನ ಶೇಕಡಾವಾರು ಹೆಚ್ಚಳ/ಕಡಿಮೆ |
| ಚನ್ನಪ್ಪಾ ಎಂ. ನರಸಣ್ಣನವರ್, ಒಂದನೇ ದರ್ಜೆ ಗುತ್ತಿಗೆದಾರರು | 1,07,79,067/– | 22.00 ಹೆಚ್ಚು | 15.89 ಹೆಚ್ಚು |

ಮೇಲ್ಕಂಡಂತೆ ಶ್ರೀ ಚನ್ನಪ್ಪಾ ಎಂ. ನರಸಣ್ಣನವರ್, ಒಂದನೇ ದರ್ಜೆ ಗುತ್ತಿಗೆದಾರರು ಇವರು ಟೆಂಡರ್‌ನಲ್ಲಿ ಅರ್ಹತೆ ಹೊಂದಿರುವ ಗುತ್ತಿಗೆದಾರರಾಗಿದ್ದು ಇವರು ನಮೂದಿಸಿದ ದರಗಳನ್ನು ಪ್ರಸಕ್ತ ಸಾಲಿನ ದರಗಳಿಗೆ ಪರಿಷ್ಕರಿಸಿದ ಟೆಂಡರ್‌ಗಿಟ್ಟ ಮೊತ್ತಕ್ಕೆ ಹೋಲಿಸಿದಾಗ ಶೇಕಡ 15.89 ರಷ್ಟು

ಹೆಚ್ಚಾಗಿದ್ದು, ಸದರಿಯವರ ಟೆಂಡರನ್ನು ಸಂದಾನದ ಮೂಲಕ ಅಂಗೀಕರಿಸಲು ಮುಖ್ಯ ಇಂಜಿನಿಯರ್, ಸಣ್ಣ ನೀರಾವರಿ ಉತ್ತರ ವಲಯ, ಬಿಜಾಪುರ ಇವರು ಮೇಲೆ (2) ರಲ್ಲಿ ಓದಲಾದ ಪತ್ರದಲ್ಲಿ ಶಿಫಾರಸ್ಸು ಮಾಡಿರುತ್ತಾರೆ.

ಈ ಟೆಂಡರನ್ನು ಸರ್ಕಾರದಲ್ಲಿ ಪರಿಶೀಲಿಸಿ ಪ್ರಸಕ್ತ ಸಾಲಿನ ದರಗಳಿಗೆ ಪರಿಷ್ಕರಿಸಿದಂತೆ ಟೆಂಡರಿಗಿಟ್ಟ ಪರಿಷ್ಕೃತ ಮೊತ್ತ ರೂ. 93,01,307/– ಗಳ ಮೇಲೆ ಶೇಕಡಾ 13.50 ರಷ್ಟು ಹೆಚ್ಚಿನ ದರಗಳಿಗೆ ಅಂದರೆ ರೂ. 1,05,56,983/–ಗಳಿಗೆ ಟೆಂಡರನ್ನು ಅನುಮೋದಿಸಲು ಪರಿಗಣಿಸಿದೆ.

ಮೇಲಿನ ಅಂಶಗಳ ಹಿನ್ನೆಲೆಯಲ್ಲಿ ಸರ್ಕಾರವು ಈ ಕೆಳಕಂಡಂತೆ ಆದೇಶ ಹೊರಡಿಸಿದೆ.

**ಸರ್ಕಾರದ ಆದೇಶ ಸಂಖ್ಯೆ : ಸನೀಇ 128 ಅಪಿಬಂ (ತಾಂತ್ರಿಕ) 2012, ಬೆಂಗಳೂರು, ದಿನಾಂಕ : 3ನೇ ಜನವರಿ, 2013.**

ಪ್ರಸ್ತಾವನೆಯಲ್ಲಿ ವಿವರಿಸಿರುವ ಅಂಶಗಳ ಹಿನ್ನೆಲೆಯಲ್ಲಿ ಬೆಳಗಾವಿ ಜಿಲ್ಲೆ ಹಾಗೂ ತಾಲ್ಲೂಕಿನ ಕಲ್ಲೆಹೊಳೆ ಗ್ರಾಮದ ಹತ್ತಿರ ಮಾರ್ಕಂಡೇಯ ನದಿಗೆ ಅಡ್ಡಲಾಗಿ ಬ್ಯಾರೇಜ್ ಕಂ ಬ್ರಿಡ್ಜ್ ನಿರ್ಮಾಣ ಕಾಮಗಾರಿಯನ್ನು ಪ್ರಸಕ್ತ ಸಾಲಿನ ದರಪಟ್ಟಿಯ ದರಗಳನ್ನು ಪರಿಗಣಿಸಿ ಪರಿಷ್ಕರಿಸಿದಂತೆ ಟೆಂಡರಿಗಿಡಲಾದ ಮೊತ್ತ ರೂ. 93,01,307/–ಗಳ ಮೇಲೆ ಶೇ. 13.50 ರಷ್ಟು ಹೆಚ್ಚಿನ ದರಗಳಿಗೆ ಅಂದರೆ ರೂ. 1,05,56,983/–ಗಳಿಗೆ (ರೂ. ಒಂದು ಕೋಟಿ ಐದು ಲಕ್ಷದ ಐವತ್ತಾರು ಸಾವಿರದ ಒಂಬೈನೂರ ಎಂಬತ್ತೂರು ಮಾತ್ರ) ಗಳಿಗೆ ಶ್ರೀ ಚನ್ನಪ್ಪಾ ಎಂ. ನರಸಣ್ಣನವರ್, ಒಂದನೇ ದರ್ಜೆ ಗುತ್ತಿಗೆದಾರರು ರವರಿಗೆ ಕೆಳಕಂಡ ಷರತ್ತುಗಳಿಗೆ ಒಳಪಡಿಸಿ ವಹಿಸಲು ಸರ್ಕಾರವು ಅನುಮೋದನೆ ನೀಡಿದೆ.

1. ಕಾಮಗಾರಿಯನ್ನು ನಿಗಧಿತ ಅವಧಿಯಲ್ಲಿ ಪೂರ್ಣಗೊಳಿಸತಕ್ಕದ್ದು.
2. ಸರ್ಕಾರದ ಅನುಮತಿ ಪಡೆಯದೆ ಕಾಮಗಾರಿಯಲ್ಲಿ ಯಾವುದೇ ಹೆಚ್ಚುವರಿ ಕೆಲಸ ನಿರ್ವಹಿಸಬಾರದು.

ಈ ಆದೇಶವನ್ನು ಆರ್ಥಿಕ ಇಲಾಖೆಯ ಆದೇಶ ಸಂಖ್ಯೆ : ಎಫ್‌ಡಿ 1 ಟಿಎಫ್‌ಪಿ 2002, ದಿನಾಂಕ : 20–1–2003 ರಲ್ಲಿ ಇಲಾಖಾ ಕಾರ್ಯದರ್ಶಿಯವರಿಗೆ ನೀಡಿರುವ ಆರ್ಥಿಕಾಧಿಕಾರದನ್ವಯ ಹೊರಡಿಸಲಾಗಿದೆ.

ಕರ್ನಾಟಕ ರಾಜ್ಯಪಾಲರ ಆದೇಶಾನುಸಾರ ಮತ್ತು ಅವರ ಹೆಸರಿನಲ್ಲಿ
**ರುದ್ರಮೂರ್ತಿ**
ಪದನಿಮಿತ್ತ ಸರ್ಕಾರದ ಅಧೀನ ಕಾರ್ಯದರ್ಶಿ,
ಜಲಸಂಪನ್ಮೂಲ ಇಲಾಖೆ (ಸಣ್ಣ ನೀರಾವರಿ).

P.R. 103

## ಜಲಸಂಪನ್ಮೂಲ ಸಚಿವಾಲಯ

**ವಿಷಯ :** ಬೆಳಗಾವಿ ಜಿಲ್ಲೆ ಹಾಗೂ ತಾಲ್ಲೂಕಿನ ರಕ್ಕಸಕೊಪ್ಪ ಗ್ರಾಮದ ಹತ್ತಿರ ಮಾರ್ಕಂಡೇಯ ನದಿಗೆ ಅಡ್ಡಲಾಗಿ ಬ್ಯಾರೇಜ್ ಕಂ ಬ್ರಿಡ್ಜ್ ನಿರ್ಮಾಣ ಕಾಮಗಾರಿಯ ಟೆಂಡರ್ ಅನುಮೋದಿಸುವ ಬಗ್ಗೆ.

**ಓದಲಾಗಿದೆ :**
1. ಸರ್ಕಾರದ ಆದೇಶ ಸಂಖ್ಯೆ : ಸನೀಇ 12 ಮಸಾವಿ 2011 (16) ತಾಂತ್ರಿಕ, ದಿನಾಂಕ: 11–8–2011.
2. ಮುಖ್ಯ ಇಂಜಿನಿಯರ್, ಸಣ್ಣ ನೀರಾವರಿ ಉತ್ತರ ವಲಯ ಬಿಜಾಪುರರವರ ಪತ್ರದ ಸಂಖ್ಯೆ: ಮುಇಂ/ಸನೀ(ಉ)ವಲಯ/ಬಿಜೆಪಿ/ಎಇ–1/2012–13/6139, ದಿನಾಂಕ : 16–11–2012

**ಪ್ರಸ್ತಾವನೆ :**

ಬೆಳಗಾವಿ ಜಿಲ್ಲೆ ಹಾಗೂ ತಾಲ್ಲೂಕಿನ ರಕ್ಕಸಕೊಪ್ಪ ಗ್ರಾಮದ ಹತ್ತಿರ ಮಾರ್ಕಂಡೇಯ ನದಿಗೆ ಅಡ್ಡಲಾಗಿ ಬ್ಯಾರೇಜ್ ಕಂ ಬ್ರಿಡ್ಜ್ ನಿರ್ಮಾಣ ಕಾಮಗಾರಿ ಅಂದಾಜಿಗೆ ಎ.ಐ.ಬಿ.ಪಿ. ಕಾರ್ಯಕ್ರಮದಡಿ ಉಲ್ಲೇಖ (1) ರಲ್ಲಿ ನಮೂದಿಸಿರುವ ಸರ್ಕಾರದ ಆದೇಶದಲ್ಲಿ ರೂ. 100.00 ಲಕ್ಷಗಳಿಗೆ ಆಡಳಿತಾತ್ಮಕ ಅನುಮೋದನೆ ನೀಡಲಾಗಿದ್ದು ಮುಖ್ಯ ಇಂಜಿನಿಯರ್, ಸಣ್ಣ ನೀರಾವರಿ ಉತ್ತರ ವಲಯ ಬಿಜಾಪುರರವರು ತಾಂತ್ರಿಕ ಮಂಜೂರಾತಿ ನೀಡಿರುತ್ತಾರೆ. ಈ ಕಾಮಗಾರಿಯನ್ನು ಕೈಗೊಳ್ಳಲು ಭಾರತ ಸರ್ಕಾರದ ಅನುಮೋದನೆ ದೊರಕಿರುತ್ತದೆ.

ಈ ಕಾಮಗಾರಿಯನ್ನು ಕೈಗೊಳ್ಳಲು ಬೆಳಗಾವಿ ಸಣ್ಣ ನೀರಾವರಿ ವಿಭಾಗದಿಂದ ಕರ್ನಾಟಕ ಸಾರ್ವಜನಿಕ ಸಂಗ್ರಹಣೆಗಳಲ್ಲಿ ಪಾರದರ್ಶಕತೆ ಅಧಿನಿಯಮದಡಿ ಇ–ಪ್ರೊಕ್ಯೂರ್‌ಮೆಂಟ್ ಮೂಲಕ ಕರೆಯಲಾದ ಟೆಂಡರ್ ಪ್ರಕಟಣೆಯನ್ನು ಕೆಳಕಂಡ ಮಾಧ್ಯಮಗಳಲ್ಲಿ ಪ್ರಕಟಿಸಲಾಗಿದೆ.

| | |
|---|---|
| ಜಿಲ್ಲಾ ಟೆಂಡರ್ ಬುಲೆಟಿನ್ | 13–8–2012 |

ದಿನಾಂಕ : 17–10–2012 ರಂದು ಇ–ಪ್ರೊಕ್ಯೂರ್‌ಮೆಂಟ್ ಮೂಲಕ ಟೆಂಡರ್‌ನ ತಾಂತ್ರಿಕ ಬಿಡ್‌ಅನ್ನು ತೆರೆದು ಪರಿಶೀಲಿಸಲಾಗಿರುತ್ತದೆ. ಈ ಟೆಂಡರ್ ಪ್ರಕಟಣೆಗೆ ಸ್ಪಂದಿಸಿ ಇಬ್ಬರು ಗುತ್ತಿಗೆದಾರರು ಭಾಗವಹಿಸಿದ್ದು ಈ ಪೈಕಿ ಒಬ್ಬರು ಗುತ್ತಿಗೆದಾರರು ಮಾತ್ರ ಅರ್ಹತೆ ಹೊಂದಿರುತ್ತಾರೆ. ಇವರ ಆರ್ಥಿಕ ಬಿಡ್‌ಅನ್ನು ದಿನಾಂಕ : 8–10–2012ರಂದು ತೆರೆಯಲಾಗಿದ್ದು ವಿವರಗಳು ಕೆಳಕಂಡಂತಿವೆ.

| | | | |
|---|---|---|---|
| ಮಂಜೂರಾದ ಅಂದಾಜಿನ ದರಗಳಂತೆ ಟೆಂಡರಿಗೆ ಇಡಲಾದ ಮೊತ್ತ | | | ರೂ. 96,53,576/– |
| ಪ್ರಸಕ್ತ ಸಾಲಿನ ದರಗಳನ್ನು ಪರಿಗಣಿಸಿ ಪರಿಷ್ಕರಿಸಿದಂತೆ ಟೆಂಡರಿಗೆ ಇಡಲಾದ ಮೊತ್ತ | | | ರೂ. 1,01,19,960/– |
| ಗುತ್ತಿಗೆದಾರರ ಹೆಸರು ಮತ್ತು ದರ್ಜೆ ಶ್ರೀ/ಮೆಸರ್ಸ್ | ಟೆಂಡರ್‌ನಲ್ಲಿ ಗುತ್ತಿಗೆದಾರರು ನಮೂದಿಸಿರುವ ದರಗಳಂತೆ ಟೆಂಡರಿನ ಮೊತ್ತ | ಮಂಜೂರಾದ ಅಂದಾಜಿನ ದರಗಳ ಮೇಲಿನ ಶೇಕಡಾವಾರು ಹೆಚ್ಚಳ/ಕಡಿಮೆ | ಪರಿಷ್ಕರಿಸಿದ ದರಗಳ ಮೇಲಿನ ಶೇಕಡಾವಾರು ಹೆಚ್ಚಳ/ಕಡಿಮೆ |
| ಎ.ಎಸ್. ಸವಸುದ್ದಿ, ಒಂದನೇ ದರ್ಜೆ ಗುತ್ತಿಗೆದಾರರು | 1,15,63,640/– | 19.79 ಹೆಚ್ಚು | 14.26 ಹೆಚ್ಚು |

ಮೇಲ್ಕಂಡಂತೆ ಶ್ರೀ ಎ.ಎಸ್. ಸವಸುದ್ದಿ, ಒಂದನೇ ದರ್ಜೆ ಗುತ್ತಿಗೆದಾರರು ಇವರು ಟೆಂಡರ್‌ನಲ್ಲಿ ಅರ್ಹತೆ ಹೊಂದಿರುವ ಗುತ್ತಿಗೆದಾರರಾಗಿದ್ದು ಇವರು ನಮೂದಿಸಿದ ದರಗಳನ್ನು ಪ್ರಸಕ್ತ ಸಾಲಿನ ದರಗಳಿಗೆ ಪರಿಷ್ಕರಿಸಿದಂತೆ ಟೆಂಡರ್‌ಗಿಟ್ಟ ಮೊತ್ತಕ್ಕೆ ಹೋಲಿಸಿದಾಗ ಶೇಕಡ 14.26 ರಷ್ಟು ಹೆಚ್ಚಾಗಿದ್ದು,

ಸದರಿಯವರ ಟೆಂಡರನ್ನು ಸಂಧಾನದ ಮೂಲಕ ಅಂಗೀಕರಿಸಲು ಮುಖ್ಯ ಇಂಜಿನಿಯರ್, ಸಣ್ಣ ನೀರಾವರಿ ಉತ್ತರ ವಲಯ, ಬಿಜಾಪುರ ಇವರು ಮೇಲೆ (2) ರಲ್ಲಿ ಓದಲಾದ ಪತ್ರದಲ್ಲಿ ಶಿಫಾರಸ್ಸು ಮಾಡಿರುತ್ತಾರೆ.

ಈ ಟೆಂಡರನ್ನು ಸರ್ಕಾರದಲ್ಲಿ ಪರಿಶೀಲಿಸಿ ಪ್ರಸಕ್ತ ಸಾಲಿನ ದರಗಳಿಗೆ ಪರಿಷ್ಕರಿಸಿದಂತೆ ಟೆಂಡರಿಗಿಟ್ಟ ಪರಿಷ್ಕೃತ ಮೊತ್ತ ರೂ. 1,01,19,960/–ಗಳ ಮೇಲೆ ಶೇಕಡಾ 13.50 ರಷ್ಟು ಹೆಚ್ಚಿನ ದರಗಳಿಗೆ ಅಂದರೆ ರೂ. 1,14,85.155/–ಗಳಿಗೆ ಟೆಂಡರನ್ನು ಅನುಮೋದಿಸಲು ಪರಿಗಣಿಸಿದೆ.

ಮೇಲಿನ ಅಂಶಗಳ ಹಿನ್ನೆಲೆಯಲ್ಲಿ ಸರ್ಕಾರವು ಈ ಕೆಳಕಂಡಂತೆ ಆದೇಶ ಹೊರಡಿಸಿದೆ.

**ಸರ್ಕಾರದ ಆದೇಶ ಸಂಖ್ಯೆ : ಸನೀಇ 129 ಅಪಿಬಂ (ತಾಂತ್ರಿಕ) 2012, ಬೆಂಗಳೂರು, ದಿನಾಂಕ : 3ನೇ ಜನವರಿ, 2013.**

ಪ್ರಸ್ತಾವನೆಯಲ್ಲಿ ವಿವರಿಸಿರುವ ಅಂಶಗಳ ಹಿನ್ನೆಲೆಯಲ್ಲಿ ಬೆಳಗಾವಿ ಜಿಲ್ಲೆ ಹಾಗೂ ತಾಲ್ಲೂಕಿನ ರಕ್ಕಸಕೊಪ್ಪ ಗ್ರಾಮದ ಹತ್ತಿರ ಮಾರ್ಕಂಡೇಯ ನದಿ ಅಡ್ಡಲಾಗಿ ಬ್ಯಾರೇಜ್ ಕಂ ಬ್ರಿಡ್ಜ್ ನಿರ್ಮಾಣ ಕಾಮಗಾರಿಯನ್ನು ಪ್ರಸಕ್ತ ಸಾಲಿನ ದರಪಟ್ಟಿಯ ದರಗಳನ್ನು ಪರಿಗಣಿಸಿ ಪರಿಷ್ಕರಿಸಿದಂತೆ ಟೆಂಡರಿಗಿಡಲಾದ ಮೊತ್ತ ರೂ. 1,01,19,960/– ಗಳ ಮೇಲೆ ಶೇಕಡಾ 13.50 ರಷ್ಟು ಹೆಚ್ಚಿನ ದರಗಳಿಗೆ ಅಂದರೆ ರೂ. 1,14,86.155/–ಗಳಿಗೆ (ರೂ. ಒಂದು ಕೋಟಿ ಹದಿನಾಲ್ಕು ಲಕ್ಷ ಎಂಬತ್ತಾರು ಸಾವಿರದ ಒಂದುನೂರ ಐವತ್ತೈದು ಮಾತ್ರ) ಗಳಿಗೆ ಶ್ರೀ ಎ.ಎಸ್. ಸವಸುದ್ದಿ, ಒಂದನೇ ದರ್ಜೆ ಗುತ್ತಿಗೆದಾರರು ರವರಿಗೆ ಕೆಳಕಂಡ ಷರತ್ತುಗಳಿಗೆ ಒಳಪಡಿಸಿ ವಹಿಸಲು ಸರ್ಕಾರವು ಅನುಮೋದನೆ ನೀಡಿದೆ.

1. ಕಾಮಗಾರಿಯನ್ನು ನಿಗಧಿತ ಅವಧಿಯಲ್ಲಿ ಪೂರ್ಣಗೊಳಿಸತಕ್ಕದ್ದು.
2. ಸರ್ಕಾರದ ಅನುಮತಿ ಪಡೆಯದೆ ಕಾಮಗಾರಿಯಲ್ಲಿ ಯಾವುದೇ ಹೆಚ್ಚುವರಿ ಕೆಲಸ ನಿರ್ವಹಿಸಬಾರದು.

ಈ ಆದೇಶವನ್ನು ಆರ್ಥಿಕ ಇಲಾಖೆಯ ಆದೇಶ ಸಂಖ್ಯೆ : ಎಫ್‌ಡಿ 1 ಟಿಎಫ್‌ಪಿ 2002, ದಿನಾಂಕ : 20–1–2003 ರಲ್ಲಿ ಇಲಾಖಾ ಕಾರ್ಯದರ್ಶಿಯವರಿಗೆ ನೀಡಿರುವ ಆರ್ಥಿಕಾಧಿಕಾರದನ್ವಯ ಹೊರಡಿಸಲಾಗಿದೆ.

ಕರ್ನಾಟಕ ರಾಜ್ಯಪಾಲರ ಆದೇಶಾನುಸಾರ ಮತ್ತು ಅವರ ಹೆಸರಿನಲ್ಲಿ
**ರುದ್ರಮೂರ್ತಿ**
ಪದನಿಮಿತ್ತ ಸರ್ಕಾರದ ಅಧೀನ ಕಾರ್ಯದರ್ಶಿ,
ಜಲಸಂಪನ್ಮೂಲ ಇಲಾಖೆ (ಸಣ್ಣ ನೀರಾವರಿ).

**P.R. 104**

## ನಗರಾಭಿವೃದ್ಧಿ ಸಚಿವಾಲಯ

**ವಿಷಯ :** ಮಡಿಕೇರಿ ನಗರಕ್ಕೆ ಒಳಚರಂಡಿ ವ್ಯವಸ್ಥೆಯನ್ನು ರೂ.6220.00 ಲಕ್ಷಗಳಲ್ಲಿ ಕೈಗೆತ್ತಿಕೊಳ್ಳಲು ಆಡಳಿತಾತ್ಮಕ ಅನುಮೋದನೆ ನೀಡುವ ಕುರಿತು.

**ಓದಲಾಗಿದೆ :** ವ್ಯವಸ್ಥಾಪಕ ನಿರ್ದೇಶಕರು, ಕನನೀಸ ಮತ್ತು ಒಚ ಮಂಡಳಿ, ಬೆಂಗಳೂರು ರವರ ಪತ್ರ ಸಂಖ್ಯೆ: ಕಜಮಂ: ತಾಂತ್ರಿಕ/ಮು.ಅ/ಆಶ್ರೇಕಾಅ–2/ತಾ.ಸ–10/ಸಅ–12/ಮಡಿಕೇರಿ/ಒ.ಚ.ಯೋ/2275/2011–12, ದಿನಾಂಕ: 18–10–2011.

**ಪ್ರಸ್ತಾವನೆ :**

ಮಡಿಕೇರಿ ನಗರವು ಕೊಡಗು ಜಿಲ್ಲೆಯ ಜಿಲ್ಲಾ ಕೇಂದ್ರವಾಗಿದ್ದು, 2001ರ ಜನಗಣತಿಯಂತೆ ಪಟ್ಟಣದ ಜನಸಂಖ್ಯೆಯು 32,286 ಇದ್ದು ಪ್ರಸ್ತುತ ಜನಸಂಖ್ಯೆ 36,915 ಇರುತ್ತದೆ. 2026ರ ಮಧ್ಯಂತರ ಅವಧಿಗೆ 47,000 ಹಾಗೂ 2041ರಲ್ಲಿ 55,000 ಜನಸಂಖ್ಯೆ ನಿರೀಕ್ಷಿಸಲಾಗಿದೆ. ಮಡಿಕೇರಿ ನಗರಕ್ಕೆ ಕೂಟುಹೊಳೆ ಜಲಾಶಯ ಮೂಲದಿಂದ 4,54 ಎಂ.ಎಲ್.ಡಿ, ಸಾಮರ್ಥ್ಯದ ನೀರು ಸರಬರಾಜು ವ್ಯವಸ್ಥೆ ಇದ್ದು, ಯೋಜನೆಯನ್ನು 2004ನೇ ಸಾಲಿನಲ್ಲಿ ಅನುಷ್ಠಾನಗೊಳಿಸಲಾಗಿದೆ. ಇದಲ್ಲದೆ ನಗರದಲ್ಲಿ ವಿದ್ಯುತ್ ಯಂತ್ರ ಅಳವಡಿಸಿರುವ ಕೊಳವೆ ಬಾವಿಗಳಿಂದ ಹಾಗೂ ತೆರೆದ ಬಾವಿಗಳಿಂದ ನೀರನ್ನು ಪಡೆಯಲಾಗುತ್ತಿದ್ದು, ಮಡಿಕೇರಿ ನಗರಕ್ಕೆ ಪ್ರಸ್ತುತ ತಲಾ ದಿನಂಪ್ರತಿ 100 ಲೀಟರ್‌ನಂತೆ ನೀರು ಸರಬರಾಜು ಮಾಡಲಾಗುತ್ತಿದ್ದು ಸದರಿ ಸರಬರಾಜನ್ನು ದಿನಂಪ್ರತಿ ತಲಾ 135 ಲೀಟರ್‌ನಂತೆ ನೀರು ಸರಬರಾಜು ಮಾಡಲು ವಿನ್ಯಾಸಿಸಿದ ರೂ.30.00 ಕೋಟಿಯ ಅಭಿವೃದ್ಧಿ ಯೋಜನೆಯು ಪ್ರಗತಿಯಲ್ಲಿರುತ್ತದೆ.

ಈ ಪಟ್ಟಣಕ್ಕೆ ಪ್ರಸ್ತುತ ಒಳಚರಂಡಿ ವ್ಯವಸ್ಥೆ ಇರುವುದಿಲ್ಲ. ಕೆಲವು ಪ್ರದೇಶಗಳಲ್ಲಿ ಮಲೀನ ನೀರನ್ನು ತೆರೆದ ಚರಂಡಿಗೆ ಹರಿಯಲು ಬಿಡುತ್ತಿದ್ದು, ಇದರಿಂದ ಮೇಲ್ಮೈ ಜಲಮೂಲ ಹಾಗೂ ಅಂತರ್ ಜಲ ನೀರು ಕಲುಷಿತಗೊಳ್ಳುತ್ತಿದ್ದು ಸಾರ್ವಜನಿಕರ ಆರೋಗ್ಯದ ಮೇಲೆ ದುಷ್ಪರಿಣಾಮ ಉಂಟಾಗುತ್ತಿದೆ. ಆದ್ದರಿಂದ ಶಾಶ್ವತ ಪರಿಹಾರಕ್ಕಾಗಿ ಈ ಪಟ್ಟಣಕ್ಕೆ ಒಳಚರಂಡಿ ವ್ಯವಸ್ಥೆ ಕಲ್ಪಿಸುವುದು ಅವಶ್ಯವಾಗಿರುತ್ತದೆ.

ವ್ಯವಸ್ಥಾಪಕ ನಿರ್ದೇಶಕರು, ಕರ್ನಾಟಕ ನಗರ ನೀರು ಸರಬರಾಜು ಮತ್ತು ಒಳಚರಂಡಿ ಮಂಡಳಿ ರವರು ಈ ಕೆಳಕಂಡ ಆರ್ಥಿಕ ಮಾದರಿಯಂತೆ ಆಡಳಿತಾತ್ಮಕ ಅನುಮೋದನೆಯನ್ನು ಕೋರಿ ಪ್ರಸ್ತಾವನೆಯನ್ನು ಸರ್ಕಾರಕ್ಕೆ ಸಲ್ಲಿಸಿರುತ್ತಾರೆ.

| | |
|---|---|
| ಕರ್ನಾಟಕ ಸರ್ಕಾರದ ಅನುದಾನ (70%) | ರೂ. 4354.00 ಲಕ್ಷಗಳು |
| ಆರ್ಥಿಕ ಸಂಸ್ಥೆಗಳಿಂದ ಸಾಲ (20%) | ರೂ. 1244.00 ಲಕ್ಷಗಳು |
| ಸ್ಥಳೀಯ ಸಂಸ್ಥೆಯ ಕೊಡುಗೆ (10%) | ರೂ. 622.00 ಲಕ್ಷಗಳು |
| **ಒಟ್ಟು** | **ರೂ. 6220.00 ಲಕ್ಷಗಳು** |

ಈ ಯೋಜನೆಯನ್ನು ಮಂಡಳಿಯ 2011–12ನೇ ಸಾಲಿನ ಅನುಮೋದಿತ ಕ್ರಿಯಾಯೋಜನೆಯಲ್ಲಿ ಸೇರಿಸಿ ರೂ.2074.00 ಲಕ್ಷಗಳನ್ನು ಅನುವು ಮಾಡಲಾಗಿದೆ.

ಯೋಜನೆಯ ಅಂದಾಜಿನಲ್ಲಿ ವಿಧಿಸಿರುವ ಇಟಿಪಿ ಮತ್ತು ಸಾದಿಲ್ವಾರು ವೆಚ್ಚಗಳನ್ನು ಶೇಕಡ 5 ಕ್ಕೆ ಮಿತಿಗೊಳಿಸಬೇಕಾಗಿರುತ್ತದೆ. ಅದರಂತೆ ಯೋಜನೆಯ ಮೂಲ ಅಂದಾಜು ಮೊತ್ತವಾದ ರೂ.4711.50 ಲಕ್ಷಗಳಿಗೆ ಶೇಕಡ 5 ರಂತೆ ಇಟಿಪಿ ಮತ್ತು ಸಾದಿಲ್ವಾರು ವೆಚ್ಚಗಳಾದ ರೂ.235.58 ಲಕ್ಷಗಳನ್ನು

ಮತ್ತು ಇತರೆ ವೆಚ್ಚಗಳಾದ ರೂ.0.92 ಲಕ್ಷಗಳು ಮತ್ತು ಇತರೆ ಠೇವಣಿಗಳಿಗೆ ರೂ.9.00 ಲಕ್ಷಗಳು ಸೇರಿ ಯೋಜನೆಯ ಅಂದಾಜನ್ನು ರೂ.4956.00 ಲಕ್ಷಗಳಿಗೆ ಮಿತಿಗೊಳಿಸಬೇಕಾಗಿರುತ್ತದೆ. ಇದಲ್ಲದೆ ಯೋಜನೆಯ ಅಂದಾಜಿನಲ್ಲಿ ಸೇರಿಸಿರುವ ಏಸ್ಕಲೇಷನ್ ದರಗಳನ್ನು, ದರಗಳ ಹೊಂದಾಣಿಕೆ ಹಾಗೂ ಭೂ ಸ್ವಾಧೀನಕ್ಕೆ ನಿಗಧಿಪಡಿಸಿರುವ ಮೊತ್ತಗಳನ್ನು ಸ್ಥಳೀಯ ಸಂಸ್ಥೆಯೇ ಭರಿಸಲು ಒಪ್ಪಿ ಠರಾವು ಪಾಸು ಮಾಡಿರುವ ಹಿನ್ನಲೆಯಲ್ಲಿ ಸದರಿ ಮೊತ್ತವನ್ನು ಅಂದಾಜು ಪಟ್ಟಿಯಿಂದ ಹೊರತುಪಡಿಸಬೇಕಾಗಿರುತ್ತದೆ. ಆದ್ದರಿಂದ ಯೋಜನೆಯ ಅಂದಾಜನ್ನು ರೂ.4956.00 ಲಕ್ಷಗಳಿಗೆ ಮಿತಿಗೊಳಿಸಬೇಕಾಗಿರುತ್ತದೆ.

ಸರ್ಕಾರವು ಪ್ರಸ್ತಾವನೆಯನ್ನು ಕೂಲಂಕಷವಾಗಿ ಪರಿಶೀಲಿಸಿ ಈ ಕೆಳಕಂಡಂತೆ ಆದೇಶಿಸಿದೆ.

**ಸರ್ಕಾರದ ಆದೇಶ ಸಂಖ್ಯೆ: ನಅಇ 23 ಯುಡಿಎಸ್ 2011 ಬೆಂಗಳೂರು, ದಿನಾಂಕ: 25–08–2012.**

ಪ್ರಸ್ತಾವನೆಯಲ್ಲಿ ವಿವರಿಸಿರುವ ಅಂಶಗಳ ಹಿನ್ನೆಲೆಯಲ್ಲಿ ಮಡಿಕೇರಿ ನಗರಕ್ಕೆ ಒಳಚರಂಡಿ ವ್ಯವಸ್ಥೆಯನ್ನು ರೂ.4956.00 ಲಕ್ಷಗಳಲ್ಲಿ (ರೂ.ನಾಲ್ಕು ಸಾವಿರದ ಒಂಬೈನೂರ ಐವತ್ತಾ ಆರು ಲಕ್ಷಗಳು ಮಾತ್ರ) ಕರ್ನಾಟಕ ನಗರ ನೀರು ಸರಬರಾಜು ಮತ್ತು ಒಳಚರಂಡಿ ಮಂಡಳಿಯು ಕೈಗೆತ್ತಿಕೊಳ್ಳಲು ಈ ಕೆಳಕಂಡ ಷರತ್ತು ಮತ್ತು ನಿಬಂಧನೆಗಳಿಗೊಳಪಟ್ಟು ಸರ್ಕಾರದ ಆಡಳಿತಾತ್ಮಕ ಅನುಮೋದನೆಯನ್ನು ನೀಡಿದೆ.

1. Since escalation and tender premium is to be met from ULB contribution, providing it separately in the project estimate is not right. This component is reduced to such extent in the estimate.
2. The board shall invite the tender immediately after the handing over of the land required if any under the scheme in order to avoid time and cost run over.
3. Adequate provision to be made by the Board in the following years for timely completion of the Project;
4. Water rates as proposed by KUWS & DB have to be implemented to meet O & M cost of UGD;
5. KTPP provisions, quality control and timely completion should ensured;
6. Board should adopt proper technology for water treatment which requires less energy and less maintenance since ULB as to mobilize large resource for its O & M;
7. ಅಂದಾಜು ಪರಿಷ್ಕರಣೆಗೆ ಯಾವುದೇ ಅವಕಾಶ ನೀಡತಕ್ಕದಲ್ಲ;
8. ಸದರಿ ಕಾಮಗಾರಿಯನ್ನು ನಿಗಧಿತ ಅವಧಿಯ ಒಳಗೆ ಪೂರ್ಣಗೊಳಿಸುವುದು;

ಈ ಆದೇಶವನ್ನು ಆರ್ಥಿಕ ಇಲಾಖೆಯ ಟಿಪ್ಪಣಿ ಸಂಖ್ಯೆ: FD 48 Exp-9:2012, ದಿನಾಂಕ:23–06–2012 ರಲ್ಲಿ ನೀಡಿರುವ ಸಹಮತಿಯನ್ವಯ ಹೊರಡಿಸಲಾಗಿದೆ.

ಕರ್ನಾಟಕ ರಾಜ್ಯಪಾಲರ ಆದೇಶಾನುಸಾರ ಮತ್ತು ಅವರ ಹೆಸರಿನಲ್ಲಿ,
**ಟಿ.ಎಂ.ವಾಸುದೇವರಾವ್,**
ಸರ್ಕಾರದ ಅಧೀನ ಕಾರ್ಯದರ್ಶಿ,
ನಗರಾಭಿವೃದ್ಧಿ ಇಲಾಖೆ.

**P.R. 144**

## ನಗರಾಭಿವೃದ್ಧಿ ಸಚಿವಾಲಯ

### ತಿದ್ದುಪಡಿ ಆದೇಶ

**ಸಂಖ್ಯೆ: ನಅಇ 14 ಯುಡಬ್ಲ್ಯೂಎಸ್ 2011, ಬೆಂಗಳೂರು, ದಿನಾಂಕ:02–11–2012.**

**ವಿಷಯ :** ಚನ್ನರಾಯಪಟ್ಟಣಕ್ಕೆ ಹೇಮಾವತಿ ನದಿ ಮೂಲದಿಂದ ಹೆಚ್ಚುವರಿ ನೀರು ಸರಬರಾಜು ಯೋಜನೆಯನ್ನು ಅಂದಾಜು ರೂ.5300.00 ಲಕ್ಷಗಳಲ್ಲಿ ಕೈಗೆತ್ತಿಕೊಳ್ಳಲು ಆಡಳಿತಾತ್ಮಕ ಅನುಮೋದನೆ ನೀಡುವ ಕುರಿತು.

**ಉಲ್ಲೇಖ :** ಸರ್ಕಾರದ ಆದೇಶ ಸಂಖ್ಯೆ:ನಅಇ 14 ಯುಡಬ್ಲ್ಯೂಎಸ್ 2011 ದಿನಾಂಕ: 09–10–2012.

ಉಲ್ಲೇಖಿತ ಸರ್ಕಾರದ ಆದೇಶದಲ್ಲಿನ ಆದೇಶ ಭಾಗದ ಮೊದಲನೆ ಸಾಲಿನಲ್ಲಿ **"ಚನ್ನಪಟ್ಟಣಕ್ಕೆ ಹೇಮಾವತಿ ನದಿ"** ಎನ್ನುವ ಬದಲಾಗಿ **"ಚನ್ನರಾಯಪಟ್ಟಣಕ್ಕೆ ಹೇಮಾವತಿ ನದಿ"** ಎಂದು ತಿದ್ದಿ ಓದಿಕೊಳ್ಳತಕ್ಕದ್ದು.

ಕರ್ನಾಟಕ ರಾಜ್ಯಪಾಲರ ಆದೇಶಾನುಸಾರ ಮತ್ತು ಅವರ ಹೆಸರಿನಲ್ಲಿ,
**ಟಿ.ಎಂ.ವಾಸುದೇವರಾವ್,**
ಸರ್ಕಾರದ ಅಧೀನ ಕಾರ್ಯದರ್ಶಿ,
ನಗರಾಭಿವೃದ್ಧಿ ಇಲಾಖೆ.

**P.R. 145**

## ಇಂಧನ ಸಚಿವಾಲಯ

**ವಿಷಯ :** ರಾಜ್ಯದಲ್ಲಿರುವ ಅನಧಿಕೃತ ನೀರಾವರಿ ಪಂಪ್‌ಸೆಟ್‌ಗಳ ಸಕ್ರಮೀಕರಣಕ್ಕಾಗಿ ವಿದ್ಯುತ್ ಸರಬರಾಜು ಕಂಪನಿಗಳಲ್ಲಿ ಮೂಲಭೂತ ಸೌಕರ್ಯ ನಿರ್ಮಾಣಕ್ಕಾಗಿ ಬಂಡವಾಳ ಹೂಡಿಕೆಗೆ ಹಣ ಬಿಡುಗಡೆ ಮಾಡುವ ಬಗ್ಗೆ.

**ಓದಲಾಗಿದೆ :** ಸರ್ಕಾರಿ ಆದೇಶ ಸಂಖ್ಯೆ : ಇಎನ್ 09 ಪಿಎಸ್‌ಆರ್ 2011, ದಿನಾಂಕ : 11–3–2011.

**ಪ್ರಸ್ತಾವನೆ :**

1. 2012–13ನೇ ಸಾಲಿನ ಆಯವ್ಯಯದ ಭಾಷಣದಲ್ಲಿ ರಾಜ್ಯದಲ್ಲಿರುವ ಅನಧಿಕೃತ ನೀರಾವರಿ ಪಂಪ್‌ಸೆಟ್‌ಗಳ ಸಕ್ರಮೀಕರಣಕ್ಕಾಗಿ ವಿದ್ಯುತ್ ಸರಬರಾಜು ಕಂಪನಿಗಳಲ್ಲಿ ಮೂಲಭೂತ ಸೌಕರ್ಯ ನಿರ್ಮಾಣಕ್ಕಾಗಿ ಬಂಡವಾಳ ಹೂಡಿಕೆಗೆ 2012–13ರಲ್ಲಿಯೂ ಸಹ ಉತ್ತೇಜನ

ಕೊಡುವುದಾಗಿ ತಿಳಿಸಿದೆ. ವಿದ್ಯುತ್ ಸರಬರಾಜು ಕಂಪನಿಗಳು ಜುಲೈ 2012ರ ಅಂತ್ಯಕ್ಕೆ 105416 ಅನಧಿಕೃತ ಪಂಪ್‌ಸೆಟ್‌ಗಳನ್ನು ಸಕ್ರಮೀಕರಣ ಮಾಡಿರುತ್ತಾರೆ. ಈ ಸಕ್ರಮೀಕರಣಕ್ಕೆ ರೂ. 263.54 ಕೋಟಿಗಳನ್ನು ಭರಿಸಬೇಕಾಗಿರುತ್ತದೆ. ಇದರಲ್ಲಿ ರೂ. 100 ಕೋಟಿಗಳನ್ನು 2011–12ನೇ ಸಾಲಿನಲ್ಲಿ ಬಿಡುಗಡೆ ಮಾಡಲಾಗಿದೆ. ಬಾಕಿ ಉಳಿದಿರುವ ರೂ. 163.54 ಕೋಟಿಗಳನ್ನು ಪ್ರಸ್ತುತ ಸಾಲಿನಲ್ಲಿ ಬಿಡುಗಡೆ ಮಾಡಬೇಕಾಗಿರುತ್ತದೆ.

2. 2012–13ನೇ ಸಾಲಿನ ಆಯವ್ಯಯದಲ್ಲಿ ವಿದ್ಯುಚ್ಛಕ್ತಿ ವಲಯದಲ್ಲಿ ಬಂಡವಾಳ ಹೂಡಿಕೆಗಾಗಿ ರೂ. 500 ಕೋಟಿಗಳನ್ನು ಒದಗಿಸಿರುತ್ತದೆ. ಈ ರೂ. 500 ಕೋಟಿಗಳಲ್ಲಿ ರೂ. 125 ಕೋಟಿಗಳನ್ನು ಕರ್ನಾಟಕ ವಿದ್ಯುತ್ ಪ್ರಸರಣ ನಿಗಮ ನಿಯಮಿತ ಮತ್ತು ಕರ್ನಾಟಕ ವಿದ್ಯುತ್ ನಿಗಮ ನಿಯಮಿತದಲ್ಲಿ ಬಂಡವಾಳ ಹೂಡಿಕೆಗಾಗಿ ಈಗಾಗಲೇ ಬಿಡುಗಡೆ ಮಾಡಲಾಗಿದೆ.

3. ಮೇಲೆ ಕ್ರಮ ಸಂಖ್ಯೆ 1ರಲ್ಲಿ ಓದಲಾದ ಸರ್ಕಾರಿ ಆದೇಶ ದಿನಾಂಕ : 11–3–2011ರಲ್ಲಿ ರಾಜ್ಯದ ಎಲ್ಲಾ ವಿದ್ಯುತ್ ಸರಬರಾಜು ಕಂಪನಿಗಳ ವ್ಯಾಪ್ತಿಯಲ್ಲಿ ಬರುವ ಅಕ್ರಮ ನೀರಾವರಿ ವಿದ್ಯುತ್ ಪಂಪ್‌ಸೆಟ್‌ಗಳನ್ನು ಸದರಿ ಆದೇಶದಲ್ಲಿ ವಿಧಿಸಿರುವ ಷರತ್ತುಗಳಿಗೊಳಪಟ್ಟು ಸಕ್ರಮಗೊಳಿಸಲು ಆದೇಶಿಸಿದೆ. ಪ್ರತಿ ಪಂಪ್‌ಸೆಟ್‌ನ ಸಕ್ರಮೀಕರಣಕ್ಕಾಗಿ ತಗಲುವ ವೆಚ್ಚದ ರೂ. 25 ಸಾವಿರಗಳನ್ನು ಸರ್ಕಾರ ಭರಿಸುವುದಾಗಿ ತಿಳಿಸಿದೆ.

4. ಈ ಅನಧಿಕೃತ ಪಂಪ್‌ಸೆಟ್‌ಗಳ ಸಕ್ರಮೀಕರಣಕ್ಕೆ ಎಲ್ಲಾ ವಿತರಣಾ ಕಂಪನಿಗಳಲ್ಲಿ ಮೂಲಭೂತ ಸೌಕರ್ಯ ನಿರ್ಮಾಣಕ್ಕಾಗಿ ರೂ. 80 ಕೋಟಿಗಳ ಬಂಡವಾಳ ಬಿಡುಗಡೆಗಾಗಿ ಪ್ರಸ್ತುತ ಆದೇಶ.

**ಸರ್ಕಾರದ ಆದೇಶ ಸಂಖ್ಯೆ : ಇಎನ್ 67 ಪಿಎಸ್‌ಆರ್ 2012, ಬೆಂಗಳೂರು, ದಿನಾಂಕ : 6–9–2012.**

1. ರಾಜ್ಯದ ಎಲ್ಲಾ ವಿತರಣಾ ಕಂಪನಿಗಳ ವ್ಯಾಪ್ತಿಯಲ್ಲಿ ದಿನಾಂಕ : 31–7–2012ರವರೆಗೆ ನೋಂದಾಯಿಸಿರುವ 10 ಅಶ್ವಶಕ್ತಿ (10 ಅಶ್ವಶಕ್ತಿ ಒಳಗೊಂಡಿರುವ) ವರೆಗಿನ ಅನಧಿಕೃತ ಪಂಪ್‌ಸೆಟ್‌ಗಳ ಸಕ್ರಮೀಕರಣಕ್ಕಾಗಿ ಮೂಲಭೂತ ಸೌಕರ್ಯ ನಿರ್ಮಾಣಕ್ಕಾಗಿ ಬಂಡವಾಳ ಒದಗಿಸಲು ರೂ. 80.00 ಕೋಟಿಗಳನ್ನು ಲೆಕ್ಕಶೀರ್ಷಿಕೆ HoA 4801-01-190-0-09 (Plan)211 ರಲ್ಲಿ ಈ ಕೆಳಕಂಡಂತೆ ವಿದ್ಯುತ್ ಸರಬರಾಜು ಕಂಪನಿಗಳಿಗೆ ಬಿಡುಗಡೆಗೊಳಿಸಿ ಆದೇಶಿಸಿದೆ.

| ಕ್ರಮ ಸಂಖ್ಯೆ | ಕಂಪನಿಗಳ ಹೆಸರು | ಬಿಡುಗಡೆಗೊಳಿಸಿರುವ ಮೊತ್ತ (ರೂ. ಕೋಟಿಗಳಲ್ಲಿ) |
|---|---|---|
| 1. | ಬೆಂಗಳೂರು ವಿದ್ಯುತ್ ಸರಬರಾಜು ಕಂಪನಿ | 20.00 |
| 2. | ಮಂಗಳೂರು ವಿದ್ಯುತ್ ಸರಬರಾಜು ಕಂಪನಿ | 15.00 |
| 3. | ಹುಬ್ಬಳ್ಳಿ ವಿದ್ಯುತ್ ಸರಬರಾಜು ಕಂಪನಿ | 20.00 |
| 4. | ಗುಲ್ಬರ್ಗಾ ವಿದ್ಯುತ್ ಸರಬರಾಜು ಕಂಪನಿ | 5.00 |
| 5. | ಚಾಮುಂಡೇಶ್ವರಿ ವಿದ್ಯುತ್ ಸರಬರಾಜು ನಿಗಮ | 20.00 |
| | **ಒಟ್ಟು ಮೊತ್ತ** | **80.00** |

2. ವಿದ್ಯುತ್ ಸರಬರಾಜು ಕಂಪನಿಗಳು ಹಣ ಸ್ವೀಕೃತ ರಶೀದಿಯ ಮೇಲೆ ಸರ್ಕಾರದ ಉಪ ಕಾರ್ಯದರ್ಶಿ, ಇಂಧನ ಇಲಾಖೆ ಇವರ ಮೇಲು ರುಜು ಪಡೆದು ಹಣವನ್ನು ಪಡೆಯತಕ್ಕದ್ದು.

3. ವಿದ್ಯುತ್ ಸರಬರಾಜು ಕಂಪನಿಗಳು ಬಿಡುಗಡೆ ಮಾಡಿದ ಮೊಬಲಗು ಸಕ್ರಮೀಕರಣದ ಮೂಲಭೂತ ಸೌಕರ್ಯಕ್ಕಾಗಿಯೇ ಬಳಸಿಕೊಂಡು, ಈ ಬಗ್ಗೆ ದೃಢೀಕರಣ (Utilization Certificate)ನ್ನು ಸರ್ಕಾರಕ್ಕೆ ಒದಗಿಸತಕ್ಕದ್ದು.

4. ಸಕ್ರಮಗೊಳಿಸುವ ಎಲ್ಲಾ 10 ಅಶ್ವಶಕ್ತಿ (10 ಅಶ್ವಶಕ್ತಿ ಒಳಗೊಂಡು) ವರೆಗಿನ ಅನಧಿಕೃತ ಪಂಪ್‌ಸೆಟ್‌ಗಳ ಪರಿವೀಕ್ಷಣೆ (ರೇಟಿಂಗ್) ಮಾಡಿ ಅದರ ಅಶ್ವಶಕ್ತಿಯನ್ನು ಖಚಿತಪಡಿಸಿಕೊಳ್ಳಬೇಕು. 10 ಅಶ್ವಶಕ್ತಿ ಮೇಲ್ಪಟ್ಟ ವಿದ್ಯುತ್ ಪಂಪ್‌ಸೆಟ್‌ಗಳಿಗೆ ವಿದ್ಯುತ್ ಪರಿವರ್ತಕ ಕೇಂದ್ರ (Distribution Transformer Centers) ಗಳಿಗೆ ಒದಲಾಗಿ ಪ್ರತಿ ಪಂಪ್‌ಸೆಟ್ಟಿಗೂ ಮೀಟರ್ ಅಳವಡಿಸುವುದು.

5. ಈ ಆದೇಶವನ್ನು ಸರ್ಕಾರಿ ಆದೇಶ ಸಂಖ್ಯೆ : ಎಫ್‌ಡಿ 04 ಟಿಎಫ್‌ಪಿ/2012, ದಿನಾಂಕ : 27–4–2012ರಲ್ಲಿ ಪ್ರದತ್ತವಾದ ಅಧಿಕಾರದನ್ವಯ ಬಿಡುಗಡೆಗೊಳಿಸಿದೆ.

ಕರ್ನಾಟಕ ರಾಜ್ಯಪಾಲರ ಆದೇಶಾನುಸಾರ ಮತ್ತು ಅವರ ಹೆಸರಿನಲ್ಲಿ
**ಕೌಸಲ್ಯಾ**
ಸರ್ಕಾರದ ಅಧೀನ ಕಾರ್ಯದರ್ಶಿ,
ಇಂಧನ ಇಲಾಖೆ.

P.R. 134

## ಕೃಷಿ ಸಚಿವಾಲಯ

**ವಿಷಯ :** ಮೈಸೂರು ಟೊಬ್ಯಾಕೊ ಕಂಪನಿಯ ಖಾಸಗಿ ಷೇರುದಾರರ ಷೇರುಗಳನ್ನು ಖರೀದಿಸುವ ಬಗ್ಗೆ.

**ಓದಲಾಗಿದೆ :** ವ್ಯವಸ್ಥಾಪಕ ನಿರ್ದೇಶಕರು, ಕೆಪೆಕ್‌ರವರ ಪತ್ರ ಸಂ. KAPPEC : 2007-2008/715, ದಿನಾಂಕ : 13–2–2008.

**ಪ್ರಸ್ತಾವನೆ :**

ಮೈಸೂರು ಟೊಬ್ಯಾಕೊ ಕಂಪನಿ (ಬೆಂಗಳೂರು–25) ಯನ್ನು ರಾಜ್ಯದಲ್ಲಿ ಸಿಗರೇಟು ತಂಬಾಕು ಬೆಳೆಯನ್ನು ಪ್ರೋತ್ಸಾಹಿಸಲು ಹಾಗೂ ರೈತರಿಗೆ ಕೃಷಿ ಪರಿಕರ ಒದಗಿಸುವ ಹಾಗೂ ಉತ್ಪನ್ನವನ್ನು ಮಾರುಕಟ್ಟೆ ಮಾಡಲು ನೆರವಾಗುವ ಉದ್ದೇಶದಿಂದ 1937ರಲ್ಲಿ ಪ್ರಾರಂಭಿಸಲಾಗಿದೆ. ಕಂಪನಿಯ ಅಧಿಕೃತ ಷೇರು ಬಂಡವಾಳ ರೂ. 100 ಲಕ್ಷವಾಗಿದ್ದು, ನೀಡಿಕೆ ಬಂಡವಾಳ ರೂ. 77,37,940 ಲಕ್ಷ ಇರುತ್ತದೆ. ಇದರಲ್ಲಿ ಕರ್ನಾಟಕ ಸರ್ಕಾರದ ಪಾಲು ಶೇಕಡ 78.21, ಕರ್ನಾಟಕ ಕೃಷಿ ಕೈಗಾರಿಕೆ ನಿಗಮದ ಪಾಲು ಶೇಕಡ 14.28 ಹಾಗೂ ಖಾಸಗಿ ಷೇರುದಾರರ ಪಾಲು ಶೇಕಡ 7.51 ಇರುತ್ತದೆ.

ಕಂಪನಿಯ ಆಡಳಿತ ಮಂಡಳಿಯಲ್ಲಿ ಸರ್ಕಾರದ ಪ್ರಧಾನ ಕಾರ್ಯದರ್ಶಿ, ಕೃಷಿ ಇಲಾಖೆ ಇವರು ಅಧ್ಯಕ್ಷರಾಗಿದ್ದು, ವ್ಯವಸ್ಥಾಪಕ ನಿರ್ದೇಶಕರು ಹಾಗೂ ಇಬ್ಬರು ಪ್ರಗತಿಪರ ರೈತರು ನಿರ್ದೇಶಕರಾಗಿರುತ್ತಾರೆ.

ಭಾರತ ಸರ್ಕಾರವು ಟೊಬ್ಯಾಕೊ ಮಂಡಳಿಯನ್ನು 1980ರಲ್ಲಿ ಪ್ರಾರಂಭ ಮಾಡಿದ್ದು ಕರ್ನಾಟಕದಲ್ಲಿ ಅದರ ಚಟುವಟಿಕೆಯನ್ನು 1983ರಲ್ಲಿ ಪ್ರಾರಂಭ ಮಾಡಲಾಯಿತು. ಇದರಿಂದ ಮೈಸೂರು ಟೊಬ್ಯಾಕೊ ಕಂಪನಿಯ ಎಲ್ಲಾ ಚಟುವಟಿಕೆಗಳ ಟೊಬ್ಯಾಕೋ ಮಂಡಳಿಗೆ ವರ್ಗಾಯಿಸಲ್ಪಟ್ಟಿದೆ. ಮೈಸೂರು ಟೊಬ್ಯಾಕೊ ಕಂಪನಿಗೆ ಹರಾಜು ಪ್ರಕ್ರಿಯೆಯಲ್ಲಿ ಭಾರಿ ನಷ್ಟವಾಗಿದ್ದು. ಕರ್ನಾಟಕ ಸರ್ಕಾರವು ಮೈಸೂರು ಟೊಬ್ಯಾಕೊ ಕಂಪನಿಗೆ ಯಾವುದೇ ಚಟುವಟಿಕೆ ಮಾಡಬಾರದೆಂದು ನಿರ್ದೇಶನ ನೀಡಿದ್ದು, ಅದರಂತೆ 1984 ರಿಂದ ಎಲ್ಲಾ ಚಟುವಟಿಕೆ ನಿಲ್ಲಿಸಲಾಗಿದೆ.

ಕಂಪನಿಯು ಬೆಂಗಳೂರಿನ ರಿಚ್‌ಮಂಡ್ ರಸ್ತೆಯಲ್ಲಿ ಮುಖ್ಯ ಕಛೇರಿಯನ್ನು ಹೊಂದಿದ್ದು ಸುಮಾರು 32779 ಚ.ಅಡಿ ಜಾಗವನ್ನು ಹೊಂದಿದೆ ಹಾಗೂ ವೈಟ್‌ಫೀಲ್ಡ್‌ನಲ್ಲಿ 11.83 ಎಕರೆ ಜಾಗವಿದ್ದು 16 ಗೋಡೌನುಗಳು, 10 ವಸತಿ ಗೃಹಗಳು ಇರುತ್ತವೆ. ಗೋಡೌನುಗಳನ್ನು ಕೇಂದ್ರೀಯ ಉಗ್ರಾಣ ನಿಗಮ ಹಾಗೂ ಕರ್ನಾಟಕ ರಾಜ್ಯ ಉಗ್ರಾಣ ನಿಗಮಕ್ಕೆ ಬಾಡಿಗೆಗಾಗಿ ನೀಡಲಾಗಿದೆ ಹಾಗೂ ಕಂಪನಿಯ ಹಿಂದಿನ ಸಿಬ್ಬಂದಿಗಳಿಗೆ ವಸತಿ ಗೃಹವನ್ನು ಬಾಡಿಗೆ ಮೇಲೆ ನೀಡಲಾಗಿದೆ ಹಾಗೂ ಬೆಂಗಳೂರಿನ ಕೇಂದ್ರ ಕಛೇರಿಯ ಅರ್ಧ ಭಾಗವನ್ನು ಕೆಪೆಕ್ ಸಂಸ್ಥೆಗೆ ಬಾಡಿಗೆಗೆ ಕೊಡಲಾಗಿದೆ.

ಕಂಪನಿಯು ಚಟುವಟಿಕೆ ನಡೆಸುತ್ತಿರುವ ಸಂದರ್ಭದಲ್ಲಿ ಸರ್ಕಾರದಿಂದ ಸಾಲ ಪಡೆದಿದ್ದು, ಅದರಲ್ಲಿ ರೂ. 153.77 ಲಕ್ಷ ಇನ್ನೂ ಬಾಕಿ ಇರುತ್ತದೆ ಹಾಗೂ ಇದರ ಮೇಲೆ ಬಡ್ಡಿ ಹಾಗೂ ಚಕ್ರ ಬಡ್ಡಿ ಹಣ ರೂ. 13.86 ಕೋಟಿ ಬಾಕಿ ಇರುತ್ತದೆ.

ಕಂಪನಿಯನ್ನು ಸಂಪೂರ್ಣ ಸರ್ಕಾರದ ಕಂಪನಿ ಮಾಡುವ ದಿಸೆಯಲ್ಲಿ ಸರ್ಕಾರವು ಕಂಪನಿಗೆ 2010ರಲ್ಲಿ ಬೆಂಗಳೂರಿನ ಹಾಗೂ ವೈಟ್‌ಫೀಲ್ಡ್‌ನ ಆಸ್ತಿಯನ್ನು ಮೌಲ್ಯ ಮಾಡಲು ಹಾಗೂ ಪ್ರತಿ ಷೇರಿನ ಮೌಲ್ಯವನ್ನು ನಿಗದಿಪಡಿಸಲು ನಿರ್ದೇಶನ ನೀಡಿರುತ್ತದೆ. ಅದರಂತೆ ಕಂಪನಿಯು ಅಧಿಕೃತ ಮೌಲ್ಯದಾರರಿಂದ ಬೆಂಗಳೂರು ಹಾಗೂ ವೈಟ್‌ಫೀಲ್ಡ್‌ನ ಆಸ್ತಿಯನ್ನು ಮೌಲ್ಯ ಮಾಡಿಸಿದ್ದು. ಪ್ರತಿ ಷೇರಿನ ಬೆಲೆಯನ್ನು ರೂ. 1089 ಎಂದು ನಿಗದಿಪಡಿಸಲಾಗಿದ್ದು, ಸರ್ಕಾರದ ಅನುಮತಿ ಪಡೆದು ಇದನ್ನು 2010ರ ವಾರ್ಷಿಕ ಮಹಾಸಭೆಯಲ್ಲಿ ಮಂಡಿಸಲಾಯಿತು. ಈ ಬಗ್ಗೆ ಖಾಸಗಿ ಷೇರುದಾರರು ಮೌಲ್ಯ ಮಾಡಿರುವುದು 1 ವರ್ಷ ಹಳೆಯದಾಗಿರುವುದರಿಂದ ಹೊಸದಾಗಿ ಮೌಲ್ಯಮಾಪನ ಮಾಡಲು ಮತ್ತು ಷೇರಿನ ಬೆಲೆಯನ್ನು ಮರು ನಿಗದಿಪಡಿಸಲು ಹಾಗೂ ಕಂಪನಿಯ ಸಾಲದ ಮೇಲೆ ಹಾಕಿರುವ ಬಡ್ಡಿ ಹಾಗೂ ಚಕ್ರಬಡ್ಡಿಯನ್ನು ಕೈಬಿಟ್ಟು ಷೇರಿನ ಹಣವನ್ನು ಮರು ನಿಗದಿಪಡಿಸಲು ಸೂಚಿಸಿರುತ್ತಾರೆ. ಅದರಂತೆ ಸರ್ಕಾರದ ಅನುಮತಿ ಪಡೆದು ಕಂಪನಿಯು ಬೆಂಗಳೂರಿನ ಹಾಗೂ ವೈಟ್‌ಫೀಲ್ಡ್‌ನ ಆಸ್ತಿಯನ್ನು ಅಧಿಕೃತ ಮೌಲ್ಯದಾರರಿಂದ ಮರು ಮೌಲ್ಯಮಾಪನ ಮಾಡಿಸಿದ್ದು, ಅದರಂತೆ ಪ್ರತಿ ಷೇರಿನ ಬೆಲೆಯನ್ನು ರೂ. 1,313ಕ್ಕೆ ನಿಗದಿಪಡಿಸಲಾಗಿದೆ. ಬಡ್ಡಿ ಹಾಗೂ ಚಕ್ರಬಡ್ಡಿ ರೂ. 13.86 ಕೋಟಿ ಬಿಟ್ಟು ಷೇರಿನ ಬೆಲೆಯನ್ನು ಸಹ ನಿಗದಿ ಮಾಡಿದ್ದು, ಅದು ರೂ. 1479 ಆಗಿರುತ್ತದೆ.

ಸರ್ಕಾರವು ಕೂಲಂಕಷವಾಗಿ ಪ್ರಸ್ತಾವನೆಯನ್ನು ಪರಿಶೀಲಿಸಿದ್ದು, ಅದರಂತೆ ಈ ಕೆಳಕಂಡ ಆದೇಶ ಹೊರಡಿಸಿದೆ.

**ಸರ್ಕಾರದ ಆದೇಶ ಸಂಖ್ಯೆ : ಕೃಇ/106/ಕೃಉಇ/2009, ಬೆಂಗಳೂರು, ದಿನಾಂಕ : 23–1–2013**

ಪ್ರಸ್ತಾವನೆಯಲ್ಲಿ ವಿವರಿಸಿರುವ ಕಾರಣಗಳ ಹಿನ್ನೆಲೆಯಲ್ಲಿ, ಮೈಸೂರು ಟೊಬ್ಯಾಕೊ ಕಂಪನಿ, ಬೆಂಗಳೂರು–25 ಇದರ ಖಾಸಗಿ ಷೇರುದಾರರ ಷೇರುಗಳನ್ನು ಖರೀದಿಸುವ ಕುರಿತು ಈ ಕೆಳಕಂಡ ಅಂಶಗಳಿಗೆ ಸರ್ಕಾರದ ಆಡಳಿತಾತ್ಮಕ ಅನುಮೋದನೆಯನ್ನು ನೀಡಿದೆ :–

- ಸರ್ಕಾರಕ್ಕೆ ಬಾಕಿಯಿರುವ ಬಡ್ಡಿ ಮತ್ತು ಚಕ್ರಬಡ್ಡಿಯನ್ನು ಮನ್ನಾ ಮಾಡದೆ ಮುಸ್ತಕದಲ್ಲಿ ಗುರುತಿಸಿರುವ ಷೇರು ದರವನ್ನು ಪ್ರತಿ ಷೇರಿಗೆ ರೂ. 1479.00 ರಂತೆ ಮಾರಾಟ ಮಾಡಲು ಖಾಸಗಿ ಷೇರುದಾರರೊಂದಿಗೆ ಪ್ರಸ್ತಾಪಿಸಲು :
- ಖಾಸಗಿ ಷೇರುಗಳನ್ನು ಖರೀದಿಸಲು ಅಗತ್ಯವಾಗಿರುವ ರೂ. 8.59 ಕೋಟಿಗಳ ಹೆಚ್ಚುವರಿ ಅನುದಾನವನ್ನು ಈ ಉದ್ದೇಶಕ್ಕಾಗಿ ಕೃಷಿ ಇಲಾಖೆಗೆ ಒದಗಿಸಲು ಮತ್ತು
- ಕೃಷಿ ಇಲಾಖೆಯು ಭೂ ಆಸ್ತಿಗಳನ್ನು ಸಾರ್ವಜನಿಕರ ಸೂಕ್ತ ಉದ್ದೇಶಕ್ಕಾಗಿ ಬಳಸಲು ಹಾಗೂ ಕರ್ನಾಟಕ ರಾಜ್ಯ ಕೃಷಿ ಉತ್ಪನ್ನಗಳ ಸಂಸ್ಕರಣಾ ಹಾಗೂ ರಫ್ತು ನಿಗಮ (ಕೆಪೆಕ್) ಸಂಸ್ಥೆಯ ಕೋರಿಕೆಯನ್ನು ಇಂತಹದೇ ಇತರೆ ಸರ್ಕಾರಿ ಇಲಾಖೆಗಳು/ಸಾರ್ವಜನಿಕ ನಿಗಮಗಳ ಕೋರಿಕೆಗಳೊಂದಿಗೆ ಪರಿಗಣಿಸಲು.

ಈ ಆದೇಶವನ್ನು ಆಂತರಿಕ ಆರ್ಥಿಕ ಸಲಹೆಗಾರರು ಟಿಪ್ಪಣಿ ಸಂ. ಸಂ:ಕೃಇ/37/ಆಂಆಸ/2012, ದಿನಾಂಕ : 27–2–2012 ಮತ್ತು ಆರ್ಥಿಕ ಇಲಾಖೆಯ ಟಿಪ್ಪಣಿ ಸಂ. FD/376/Exp-4/2009, ದಿನಾಂಕ : 22–9–2012ರಲ್ಲಿ ನೀಡಿರುವ ಸಹಮತಿ ಹಾಗೂ ಸಚಿವ ಸಂಪುಟ ಪ್ರಕರಣ ಸಂ. ಸಿ/785/ 2012, ದಿನಾಂಕ : 3–1–2012ರ ಅನುಮೋದನೆಯನ್ವಯ ಹೊರಡಿಸಲಾಗಿದೆ.

ಕರ್ನಾಟಕ ರಾಜ್ಯಪಾಲರ ಆದೇಶಾನುಸಾರ ಮತ್ತು ಅವರ ಹೆಸರಿನಲ್ಲಿ
**ಜೆ.ಆರ್. ವಿಶ್ವನಾಥಾಚಾರ್,**
ಸರ್ಕಾರದ ಅಧೀನ ಕಾರ್ಯದರ್ಶಿ,
ಕೃಷಿ ಇಲಾಖೆ (ಯೋಜನೆ).

P.R. 224

## INFORMATION TECHNOLOGY BIOTECHNOLOGY SCIENCE AND TECHNOLOGY SECRETARIAT

**Sub :** Constitution of AVGC Expert Panel on Development of Human Resources-Reg.

**Read :** Government Order No. ITD 23 MDA 2009, dated 7th January, 2012.

**Preamble :**

In the Government Order dt. 7th January, 2012 read above the Karnataka Animation, Visual Effects, Gaming and Comics Policy was announced. One of the objectives of the said policy is to encourage and support appropriate manpower development to bridge the demand and supply gap of Human Resources in the AVGC Sector. Para 6 of the Policy provides for setting up an AVGC Expert Panel comprising of experienced AVGC industry professionals. The Expert Panel shall study, research and report on the current trends and future requirements of the AVGC industry particularly with respect to standardization of training, internship and mentoring programs to be initiated. The Expert Panel will submit recommendations for introduction and development of standardized AVGC curriculum in Pre-University and Technical Courses ; Graduation, Diploma and Post graduation levels in the Universities.

In pursuance of the provisions of the policy, Government in consultation with Association of Bangalore Animation Industry (ABAI) and eminent personalities from the sector has decided to constitute the AVGC Expert Panel on development of Human Resources. Hence the order.

**GOVERNMENT ORDER NO. ITD 08 MIS 2013, BANGALORE DATED 10TH JANUARY, 2013.**

In the circumstances explained above, Government is pleased to constitute the "AVGC Expert Panel on Development of Human Resources" with the following :

| | | |
|---|---|---|
| 1. Mr. Biren Ghose<br>President, ABAI & Country Head, Technicolor, | - | Chairman |
| 2. Dr. Geetha Naryanan<br>Founder-Director Srishti School Art, Design & Technology | - | Member |
| 3. Dr. Bibhudutta Baral<br>Centre Head, R&D Campus NID-Bangalore | - | Member |
| 4. Mr. Ashish Kulkarni<br>CEO-BIG Animation | - | Member |
| 5. Mr. Anand Sudarshan<br>Director-Manipal Global Education Services | - | Member |
| 6. Mr. Adi Shayan<br>Studio Head-Dreamworks Dedicated Unit at Technicolor India | - | Member |
| 7. Mr. Dinesh Damodaran<br>Head-M & E –Jain Animation School | - | Member |
| 8. Mr. Deepankar Bhattacharyya<br>Head-Education Initiative – Autodesk | - | Member |
| 9. Mr. Hanif Mohammed<br>Director-Corporate Affairs-Asian Institute of Gaming and Animation (AIGA) | - | Member |
| 10. Dr. Sandhya Chintala<br>Executive Director-Sector Skill Council-NASSCOM | - | Member |
| 11. Mr. Nagarajan<br>COO-Visual Computing Labs (VCL), Tata Elxsi | - | Member |
| 12. Mr. Suresh Seetharaman<br>Founder Director-Liquid Comics | - | Member |
| 13. Director-IT&BT and<br>MD-KBITS, GoK | - | Member Secretary |

The AVGC, Expert Panel shall make recommendations regarding standardization of training, Internship and mentoring programs to be initiated for providing industry ready professionals of hish caliber required by the AVGC sector. The Expert Panel will also recommend introduction of appropriate AVGC curriculum at the Pre-University and Technical Courses level as well as at the Diploma, Graduation and Post graduation, University level. Expert Panel will also suggest a standardized evaluation mechanism and appropriate certification for evaluation and placement purposes.

Director-IT&BT and MD-KBITS shall provide the necessary secretariat services to the AVGC Expert Panel.

By Order and in the name of the Governor of Karnataka,

**E. RAMAKRISHNAPPA**

Under Secretary to Government,

IT, BT and S & T Department.

**P.R. 229**

## ಶಿಕ್ಷಣ ಸಚಿವಾಲಯ

**ವಿಷಯ :** ಶ್ರೀ ವೆಂಕಯ್ಯ ಇನಾಮದಾರ, ಹಿರಿಯ ಸಹಾಯಕ ನಿರ್ದೇಶಕರು ಆಯುಕ್ತರ ಕಛೇರಿ, ಸಾರ್ವಜನಿಕ ಶಿಕ್ಷಣ ಇಲಾಖೆ, ಗುಲ್ಬರ್ಗಾ ಮತ್ತು ಪ್ರಭಾರಿ ಕ್ಷೇತ್ರ ಶಿಕ್ಷಣಾಧಿಕಾರಿ, ಯಾದಗಿರಿ ಇವರ ವಿರುದ್ಧ ದಾಖಲಾಗಿರುವ ಟ್ರ್ಯಾಪ್ ಪ್ರಕರಣದಲ್ಲಿ ಅಭಿಯೋಜನಾ ಮಂಜೂರಾತಿ ನೀಡುವ ಬಗ್ಗೆ.

**ಓದಲಾಗಿದೆ :**
1. ಅಪರ ಪೊಲೀಸ್ ಮಹಾ ನಿರ್ದೇಶಕರು, ಕರ್ನಾಟಕ ಲೋಕಾಯುಕ್ತ, ಬೆಂಗಳೂರು ಇವರ ಪತ್ರ ಸಂಖ್ಯೆ : ಲೋಕ್/ಐಎನ್‌ವಿ(ಜಿ)/ಜಿ–70/ಸಿಆರ್ 14/2011 ಗುಲ್ಬರ್ಗಾ, ದಿನಾಂಕ : 25–10–2012.
2. ತನಿಖಾಧಿಕಾರಿಯವರ ಅಂತಿಮ ವರದಿ
3. ತನಿಖಾ ದಾಖಲೆಗಳ ನಕಲುಗಳಾದ ಫಿರ್ಯಾದು, ಪ್ರಥಮ ವರ್ತಮಾನ ಪತ್ರ ಪ್ರಾಯೋಗಿಕ ಪಂಚನಾಮೆ, ಹಣ ಜಪ್ತಿ ಪಂಚನಾಮೆ, ಸ್ವತ್ತುಗಳ ಪಟ್ಟಿ, ರಾಸಾಯನಿಕ ಪರೀಕ್ಷಕರ ವರದಿ, ಸಾಕ್ಷಿದಾರರ ಹೇಳಿಕೆಗಳು, ಲಂಚದ ಬೇಡಿಕೆಗೆ ಸಂಬಂಧಪಟ್ಟ ದಾಖಲೆಗಳು.

**ಪ್ರಸ್ತಾವನೆ :**

ಮೇಲೆ ಓದಲಾದ ಕ್ರಮಾಂಕ (1) ದಿನಾಂಕ : 25–10–2012ರ ಪತ್ರದಲ್ಲಿ ಶ್ರೀ ವೆಂಕಯ್ಯ ಇನಾಮದಾರ, ಹಿರಿಯ ಸಹಾಯಕ ನಿರ್ದೇಶಕರು ಆಯುಕ್ತರ ಕಛೇರಿ, ಸಾರ್ವಜನಿಕ ಶಿಕ್ಷಣ ಇಲಾಖೆ, ಗುಲ್ಬರ್ಗಾ ಮತ್ತು ಪ್ರಭಾರಿ ಕ್ಷೇತ್ರ ಶಿಕ್ಷಣಾಧಿಕಾರಿ, ಯಾದಗಿರಿ ಇವರ ವಿರದ್ಧ ಅಪರ ಪೊಲೀಸ್ ಮಹಾ ನಿರ್ದೇಶಕರು, ಪೊಲೀಸ್ ವಿಭಾಗ, ಕರ್ನಾಟಕ ಲೋಕಾಯುಕ್ತ, ಬೆಂಗಳೂರು, ಇವರು ಮೇಲೆ ಓದಲಾದ ಕ್ರಮಾಂಕ (2) ಮತ್ತು (3)ರಂತೆ ಯಾದಗಿರಿ ಲೋಕಾಯುಕ್ತ ಠಾಣೆ ಗುನ್ನೆ ಸಂಖ್ಯೆ: 08/2011ರಲ್ಲಿ ಪೊಲೀಸ್ ಇನ್ಸ್‌ಪೆಕ್ಟರ್, ಪೊಲೀಸ್ ವಿಭಾಗ, ಕರ್ನಾಟಕ ಲೋಕಾಯುಕ್ತ, ಯಾದಗಿರಿ ಇವರು ದಾಖಲಿಸಿರುವ ಹಾಗೂ ಗುಲ್ಬರ್ಗಾ ಪೊಲೀಸ್ ಠಾಣೆಗೆ ವರ್ಗಾವಣೆಗೊಂಡ ಗುನ್ನೆ ಸಂಖ್ಯೆ : 14/2011ರ ಪ್ರಕರಣದ ತನಿಖಾಧಿಕಾರಿಯ ಅಂತಿಮ ವರದಿಯ ನಕಲು ಮತ್ತು ತನಿಖಾ ದಾಖಲಾತಿಗಳನ್ನು ಕಳುಹಿಸಿ, ಆಪಾದಿತರನ್ನು ಘನ ನ್ಯಾಯಾಲಯದಲ್ಲಿ ಅಭಿಯೋಜನೆಗೆ ಒಳಪಡಿಸಲು ಲಂಚ ನಿರೋಧಕ ಕಾಯ್ದೆ 1988ರ ಕಲಂ 19(1)(ಬಿ)ರ ಅನ್ವಯ ಮಂಜೂರಾತಿಗಾಗಿ ಸರ್ಕಾರವನ್ನು ಕೋರಿರುತ್ತಾರೆ.

ಸಕ್ಷಮ ಪ್ರಾಧಿಕಾರಿಯಾದ ಸರ್ಕಾರವು ಅಪರ ಪೊಲೀಸ್ ಮಹಾ ನಿರ್ದೇಶಕರು, ಕರ್ನಾಟಕ ಲೋಕಾಯುಕ್ತ, ಬೆಂಗಳೂರು, ಇವರು ತಮ್ಮ ಪತ್ರ ಸಂಖ್ಯೆ : ಲೋಕ್ /ಐಎನ್‌ವಿ (ಜಿ)/ಜಿ–70/ಸಿಆರ್ 14/2011 ಗುಲ್ಬರ್ಗಾ ದಿನಾಂಕ : 25–10–2012 ರೊಂದಿಗೆ ಕಳುಹಿಸಿಕೊಟ್ಟ ಈ ಕೆಳಕಂಡ ದಾಖಲಾತಿಗಳನ್ನು ಪರಿಶೀಲಿಸಿದೆ.

1. ಫಿರ್ಯಾದಿ ಸದಾಶಿವ ರೆಡ್ಡಿ ತಂದೆ ಬಸವರಾಜಪ್ಪ ಪಾಟೀಲ್ ಬಿಳ್ಹಾರ, ಶಹಾಪುರ ತಾಲ್ಲೂಕು, ಯಾದಗಿರಿ ಜಿಲ್ಲೆ ರವರ ಸ್ವಲಿಖಿತ ದೂರಿನ ದಿನಾಂಕ : 28–7–2011.
2. ಯಾದಗಿರಿ ಲೋಕಾಯುಕ್ತ ಪೊಲೀಸ್ ಠಾಣೆ ಗುನ್ನೆ ಸಂಖ್ಯೆ : 08/2011 ಕಲಂ 7, 13(1)(ಡಿ) ಸಹಿತ 13(2) ಲಂಚ ಪ್ರತಿಬಂಧಕ ಕಾಯ್ದೆ–1988 ಪ್ರಥಮ ವರ್ತಮಾನ ವರದಿ ದಿನಾಂಕ : 28–7–2011.
3. ಗುಲ್ಬರ್ಗಾ ಲೋಕಾಯುಕ್ತ ಠಾಣೆ ಗುನ್ನೆ ಸಂಖ್ಯೆ : 14/2011 ಕಲಂ 13(2) ಲಂಚ ಪ್ರತಿಬಂಧಕ ಕಾಯ್ದೆ–1988 ಪ್ರಥಮ ವರ್ತಮಾನ ವರದಿ ದಿನಾಂಕ : 1–12–2011 (ಯಾದಗಿರಿ, ಕರ್ನಾಟಕ ಲೋಕಾಯುಕ್ತ ಪೊಲೀಸ್ ಠಾಣೆಯಿಂದ ವರ್ಗವಾಗಿ ಬಂದದ್ದು).
4. ಪ್ರಾಯೋಗಿಕ ಪಂಚನಾಮೆ (ಎಂಟ್ರಸ್ಟ್‌ಮೆಂಟ್ ಮಹಜರ್) ದಿನಾಂಕ : 28–7–2011.
5. ಹಣ ಜಪ್ತಿ ಪಂಚನಾಮೆ (ಟ್ರ್ಯಾಪ್ ಮಹಜರ್) ದಿನಾಂಕ : 28–7–2011.
6. ಸಹಾಯಕ ರಸಾಯನಿಕ ಪರೀಕ್ಷಕರು, ಸಾರ್ವಜನಿಕ ಆರೋಗ್ಯ ಸಂಸ್ಥೆ, ಬೆಂಗಳೂರು ಇವರ ವರದಿ ಪತ್ರ ಸಂಖ್ಯೆ : PHI/CME/LOK/88/11–12, ದಿನಾಂಕ : 17–8–2011.
7. ಕೃತ್ಯ ನಡೆದ ಸ್ಥಳದ ನಕಾಶೆ.
8. ಸಾಕ್ಷಿಗಳ ಹೇಳಿಕೆಗಳು :
   1. ಶ್ರೀ ಸದಾಶಿವ ರೆಡ್ಡಿ ತಂದೆ ಬಸವರಾಜಪ್ಪ ಪಾಟೀಲ್ ಬಿಳ್ಹಾರ, ಶಹಾಪುರ ತಾಲ್ಲೂಕು, ಯಾದಗಿರಿ ಜಿಲ್ಲೆ (ಫಿರ್ಯಾಧಿದಾರರು)
   2. ಶ್ರೀ ರೇವಪ್ಪ ತಂದೆ ಅಣ್ಣರಾವ ತೆಗ್ಗಿನಮನಿ ಎಫ್.ಡಿ.ಎ. ಸಹಾಯಕ ಆಯುಕ್ತರ ಕಛೇರಿ, ಯಾದಗಿರಿ ಕುಸನೂರು ಗುಲ್ಬರ್ಗಾ (ಪಂಚ ಸಾಕ್ಷಿ)
   3. ಶ್ರೀ ಸೂಗುರಪ್ಪ ತಂದೆ ತಿಪ್ಪಣ್ಣ ಕಾವಲಿ, ಜೂನಿಯರ್ ಹೆಲ್ತ್ ಅಸಿಸ್ಟೆಂಟ್, ಜಿಲ್ಲಾ ಮಲೇರಿಯಾ ಅಧಿಕಾರಿಗಳ ಕಾರ್ಯಾಲಯ, ಯಾದಗಿರಿ, ಕಡೆಚೂರು, ಯಾದಗಿರಿ (ಪಂಚ ಸಾಕ್ಷಿ)
   4. ಶ್ರೀಮತಿ ಸಿದ್ದಮ್ಮ ಗಂಡ ಮಲ್ಲಪ್ಪ ಪೂಜಾರಿ, ಗೋಡಿಹಾಳ, ಶಹಾಪುರ ತಾಲ್ಲೂಕು, ಯಾದಗಿರಿ ಜಿಲ್ಲೆ.
   5. ಶ್ರೀಮತಿ ಶರಣಮ್ಮ ಗಂಡ ಮರೆಪ್ಪ ಪೂಜಾರಿ, ಗೋಡಿಹಾಳ, ಶಹಾಪುರ ತಾಲ್ಲೂಕು, ಯಾದಗಿರಿ ಜಿಲ್ಲೆ.
   6. ಶ್ರೀ ಗುರುಶಾಂತಯ್ಯ ತಂದೆ ವೀರಯ್ಯ ಹಿರೇಮಠ, ಶಿಕ್ಷಕರು, ಟೀಚರ್ಸ್ ಕಾಲೋನಿ, ಜೇವರ್ಗಿ, ಗುಲ್ಬರ್ಗಾ
   7. ಶ್ರೀ ಬಸವರಾಜಪ್ಪ ತಂದೆ ಗಣಪತರಾವ್ ಮಲಗಂಡ, ಟೀಚರ್ಸ್ ಕಾಲೋನಿ, ಜೇವರ್ಗಿ, ಗುಲ್ಬರ್ಗಾ.
   8. ಶ್ರೀ ಜಿಲಾನಿ ತಂದೆ ಮೆಹತಾ ಹುಸೇನ, ಐ.ಬಿ.ಯಲ್ಲಿ ವಾಚಮೆನ್, ಲೋಕೋಪಯೋಗಿ ಉಪ ವಿಭಾಗ, ಜೇವರ್ಗಿ ಮುಜಂಪೂರ, ಸುರಪುರ, ಗುಲ್ಬರ್ಗಾ.
   9. ಶ್ರೀ ಶರಣಪ್ಪ ತಂದೆ ವೀರಭದ್ರಪ್ಪ ಹೂಗಾರ ಪತ್ರಾಂಕಿತ ವ್ಯವಸ್ಥಾಪಕರು, ಕ್ಷೇತ್ರ ಶಿಕ್ಷಣಾಧಿಕಾರಿ ಕಛೇರಿ, ಯಾದಗಿರಿ, ವಿಶ್ವನಗರ ಸೇಡಂ, ಗುಲ್ಬರ್ಗಾ.

10. ಶ್ರೀ ಮಜರ ಹುಸೇನ, ತಂದೆ ದಿ॥ ಆರ್. ಗುಲಾಮ ಹುಸೇನ್ ಕ್ಷೇತ್ರ ಶಿಕ್ಷಣಾಧಿಕಾರಿ, ಯಾದಗಿರಿ, ಹರಿಹರ, ದಾವಣಗೆರೆ.
11. ಶ್ರೀ ಮಧುಸೂದನ ರೆಡ್ಡಿ ತಂದೆ ರಾಮಕೃಷ್ಣ ರೆಡ್ಡಿ ಗವಿನೊಳ, ಅಧೀಕ್ಷಕರು, ಕ್ಷೇತ್ರ ಶಿಕ್ಷಣಾಧಿಕಾರಿಗಳ ಕಛೇರಿ, ಯಾದಗಿರಿ
12. ಶ್ರೀ ಸೈಯದ್ ಅಬ್ದುಲ್ ರಬ್ ತಂದೆ ಸೈಯದ್ ಗೌಸ್, ಮುಖ್ಯ ಕಾರ್ಯನಿರ್ವಾಹಕಾಧಿಕಾರಿ, ಜಿಲ್ಲಾ ಪಂಚಾಯತ್, ಯಾದಗಿರಿ, ಖಾಧರಿ ಚೌಕ್, ಆಳಂದ ರಸ್ತೆ, ಗುಲ್ಬರ್ಗಾ
13. ಶಾಂತಪ್ಪ ಜಾಧವ, ಕಿರಿಯ ಇಂಜಿನಿಯರ್, ಲೋಕೋಪಯೋಗಿ ಬಂದರು, ಒಳನಾಡು ಜಲ ಸಾರಿಗೆ ಇಲಾಖೆ, ಉಪ–ವಿಭಾಗ, ಜೇವರ್ಗಿ, ತೀರ್ಥ, ಆಳಂದ, ಗುಲ್ಬರ್ಗಾ.
14. ಶ್ರೀ ಶ್ರೀನಿವಾಸ, ಸಿ.ಹೆಚ್.ಸಿ. ಕರ್ನಾಟಕ ಲೋಕಾಯುಕ್ತ ಠಾಣೆ, ಯಾದಗಿರಿ.
15. ಶ್ರೀ ಮುತ್ತಪ್ಪ, ಸಿ.ಪಿ.ಸಿ. ಕರ್ನಾಟಕ ಲೋಕಾಯುಕ್ತ ಠಾಣೆ, ಯಾದಗಿರಿ ಇವರ ಹೇಳಿಕೆ
16. ಶ್ರೀ ಸೈಯದ್ ಶಫಿಯೋದ್ದಿನ್, ಸಿ.ಪಿ.ಸಿ. ಕರ್ನಾಟಕ ಲೋಕಾಯುಕ್ತ ಠಾಣೆ, ಯಾದಗಿರಿ ಇವರ ಹೇಳಿಕೆ
17. ಶ್ರೀ ಮಹಮ್ಮದ್ ಗೌಸ್, ಸಿ.ಪಿ.ಸಿ. ಕರ್ನಾಟಕ ಲೋಕಾಯುಕ್ತ ಠಾಣೆ, ಯಾದಗಿರಿ
18. ಶ್ರೀ ನಾಗರಾಜ, ಸಿ.ಪಿ.ಸಿ. ಕರ್ನಾಟಕ ಲೋಕಾಯುಕ್ತ ಠಾಣೆ, ಯಾದಗಿರಿ ಇವರ ಹೇಳಿಕೆ.
19. ಶ್ರೀ ವಿಜಯಕುಮಾರ, ಸಿ.ಪಿ.ಸಿ. ಕರ್ನಾಟಕ ಲೋಕಾಯುಕ್ತ ಠಾಣೆ, ಯಾದಗಿರಿ
20. ಶ್ರೀ ರಾಜಪ್ಪ, ಎ.ಪಿ.ಸಿ. ಕರ್ನಾಟಕ ಲೋಕಾಯುಕ್ತ ಠಾಣೆ, ಯಾದಗಿರಿ
21. ಶ್ರೀ ಪಾಂಡುರಂಗ, ಸಿ.ಪಿ.ಸಿ. ಕರ್ನಾಟಕ ಲೋಕಾಯುಕ್ತ ಠಾಣೆ, ಗುಲ್ಬರ್ಗಾ
22. ಶ್ರೀ ಪ್ರದೀಪಕುಮಾರ, ಸಿ.ಪಿ.ಸಿ. ಕರ್ನಾಟಕ ಲೋಕಾಯುಕ್ತ ಠಾಣೆ, ಗುಲ್ಬರ್ಗಾ,
23. ಶ್ರೀ ಇನಾಯತ್ ರೆಹಮಾನ್ ತಂದೆ ಅಬ್ದುಲ್ ರೆಹಮಾನ್ ಡೆಪ್ಯೂಟಿ ಪ್ರಾಜೆಕ್ಟ್ ಕೋ–ಆರ್ಡಿನೇಟರ್, ಡಿ.ಡಿ.ಪಿ.ಐ., ಕಛೇರಿ, ಯಾದಗಿರಿ
24. ಶ್ರೀ ಮಹಾಂತಗೌಡ, ಡಿ.ಡಿ.ಪಿ.ಐ. ಸಾರ್ವಜನಿಕ ಶಿಕ್ಷಣ ಇಲಾಖೆ, ಯಾದಗಿರಿ.

9. **ಲಂಚ ಕೇಳಲು ಆಧಾರವಾದ ಕಡತ :–** ಗೊಡಿಹಾಳ ಗ್ರಾಮದ ತುಳಸಿ ಸ್ತ್ರಿ ಶಕ್ತಿ ಸಂಘದ ಅಧ್ಯಕ್ಷರಾದ ಶ್ರೀಮತಿ ಸಿದ್ದಮ್ಮ ಗಂಡ ಮರೆಪ್ಪ ಮತ್ತು ಕಾರ್ಯದರ್ಶಿ ಶ್ರೀಮತಿ ಶರಣಮ್ಮ ಇವರು ಸರ್ಕಾರದಿಂದ ಶಾಲೆಯಿಂದ ಹೊರಗುಳಿದ ಮಕ್ಕಳಿಗಾಗಿ ಗೃಹ ಆಧಾರಿತ ಶಿಕ್ಷಣ ಕಾರ್ಯತಂತ್ರ ಯೋಜನೆ ಮಂಜೂರು ಮಾಡಿಸಿಕೊಂಡು ಬರಲು ಪ್ರಕರಣದ ಫಿರ್ಯಾದಿ ಶ್ರೀ ಸದಾಶಿವರೆಡ್ಡಿ ತಂದೆ ಬಸವರಾಜಪ್ಪ ಪಾಟೀಲ ಇವರಿಗೆ ಕೇಳಿಕೊಂಡಿದ್ದರಿಂದ ಸದರಿ ಶ್ರೀ ಸದಾಶಿವರೆಡ್ಡಿ ಇವರು ಈ ಸ್ತ್ರಿ ಶಕ್ತಿ ಸಂಘದ ಲೆಟರ್ ಪ್ಯಾಡ್‌ನಲ್ಲಿ ಸಂಘದವರ ಸಹಿ ಪಡೆದುಕೊಂಡು ಯಾದಗಿರಿ ಕ್ಷೇತ್ರ ಶಿಕ್ಷಣಾಧಿಕಾರಿಗಳ ಕಛೇರಿಗೆ ಹೋಗಿ ಇನ್‌ಚಾರ್ಜ್ ಶಿಕ್ಷಣಾಧಿಕಾರಿಗಳಾದ ಶ್ರೀ ವೆಂಕಯ್ಯ ಇನಾಮಾದಾರ (ಎಜಿಬ) ಇವರಿಗೆ ಭೇಟಿಯಾಗಿ 2011–12ನೇ ಸಾಲಿನ ಗೃಹ ಆಧಾರಿತ ಶಿಕ್ಷಣ ಕಾರ್ಯತಂತ್ರ ಯೋಜನೆ ಮಂಜೂರು ಮಾಡಿಕೊಡಲು ಕೇಳಿಕೊಂಡಾಗ ಸದರಿ ವೆಂಕಯ್ಯ ಇನಾಮಾದಾರ ಇವರು ರೂ. 50,000/– ಲಂಚ ಕೇಳಿದ್ದು ಅದಕ್ಕೆ ಚೌಕಾಸಿ ಮಾಡಿ ರೂ. 30,000/– ಲಂಚ ಕೊಡಲು ಒಪ್ಪಿಕೊಂಡು ಅದರಲ್ಲಿ ರೂ. 22,000/– ಲಂಚದ ಹಣ ಕೊಟ್ಟಾಗ ಅವರು ಇ–ಸ್ಟಾಂಪ್ ಬಾಂಡ್ ಪೇಪರ್ ಮೇಲೆ ಸಹಿ ಮಾಡಿದ್ದು ಒಡಂಬಡಿಕೆ ಪತ್ರ ಮೇಲೆ ಸಹಿ ಮಾಡಿಕೊಡಲು ಕೇಳಿದಾಗ ಇನ್ನುಳಿದ ಹಣ ಕೊಟ್ಟಾಗ ಸಹಿ ಮಾಡಿಕೊಡುವುದಾಗಿ ಹೇಳಿರುತ್ತಾರೆ. ಒಂದು ತಿಂಗಳ ನಂತರ ಯಾದಗಿರಿ ಕ್ಷೇತ್ರ ಶಿಕ್ಷಣಾಧಿಕಾರಿ ಕಛೇರಿಗೆ ಹೋಗಿ ವಿಚಾರಿಸಿದಾಗ ಬಿಇಒ ಶ್ರೀ ಮಜರ ಹುಸೇನ್ ಇವರು ಸದರಿ ಒಡಂಬಡಿಕೆ ಪತ್ರಕ್ಕೆ ಈ ಹಿಂದೆ ಇನ್–ಚಾರ್ಜ್ ಇದ್ದ ವೆಂಕಯ್ಯ ಇನಾಮಾದಾರ ಇವರೇ ಸಹಿ ಮಾಡಬೇಕಾಗುತ್ತದೆ ಎಂದು ಹೇಳಿದಾಗ ಫಿರ್ಯಾದಿಯವರು ಇನಾಮದಾರರವರ ಹತ್ತಿರ ಹೋಗಿ ಒಡಂಬಡಿಕೆ ಪತ್ರಕ್ಕೆ ಸಹಿಮಾಡಲು ಕೇಳಿಕೊಂಡಾಗ ರೂ. 5,000/– ಲಂಚದ ಹಣ ಕೊಟ್ಟರೆ ಮಾತ್ರ ಸಹಿ ಮಾಡುವುದಾಗಿ ಹೇಳಿದಾಗ ಫಿರ್ಯಾದಿ ಲಂಚದ ಹಣ ಕೊಡಲು ಮನಸ್ಸಿಲ್ಲದ ಕಾರಣ ದಿನಾಂಕ: 21–7–2011ರಂದು ಲೋಕಾಯುಕ್ತ ಠಾಣೆ ಯಾದಗಿರಿ ಕಛೇರಿಗೆ ಬಂದು ಲಂಚ ಕೇಳಿರುವ ವಿಷಯವನ್ನು ತಿಳಿಸಿ ತನಿಖಾಧಿಕಾರಿಯವರಿಗೆ ಮೌಖಿಕವಾಗಿ ತಿಳಿಸಿರುತ್ತಾರೆ. ಹಾಗೂ ದಿನಾಂಕ : 28–7–2011 ರಂದು ಸ್ವಲಿಖಿತ ದೂರನ್ನು ಸಲ್ಲಿಸಿರುತ್ತಾರೆ.

10. **ಆಪಾದಿತರ ಸಮಜಾಯಿಷಿ ಹೇಳಿಕೆ ದಿನಾಂಕ: 28–7–2011 :–** ಆಪಾದಿತ ಅಧಿಕಾರಿ ಶ್ರೀ ವೆಂಕಯ್ಯ ಇನಾಮದಾರ, ಹಿರಿಯ ಸಹಾಯಕ ನಿರ್ದೇಶಕರು ಆಯುಕ್ತರ ಕಛೇರಿ, ಸಾರ್ವಜನಿಕ ಶಿಕ್ಷಣ ಇಲಾಖೆ, ಗುಲ್ಬರ್ಗಾ ಮತ್ತು ಪ್ರಭಾರಿ ಕ್ಷೇತ್ರ ಶಿಕ್ಷಣಾಧಿಕಾರಿ, ಯಾದಗಿರಿ ರವರು ತಮ್ಮ ವಿವರಣೆಯನ್ನು ಸ್ವತಃ ಬರೆದುಕೊಟ್ಟಿದ್ದು, ಶ್ರೀ ವೆಂಕಯ್ಯ ಇನಾಮಾದಾರ, ಶಿಕ್ಷಣಾಧಿಕಾರಿಗಳು ಆಯುಕ್ತರ ಕಾರ್ಯಾಲಯ, ಗುಲ್ಬರ್ಗಾ ಇದ್ದು, ದಿನಾಂಕ : 28–7–2011 ರಂದು ತಾನು ತನ್ನ ಮನೆಯಲ್ಲಿ ಇರುವಾಗ (ಅಂದರೆ ಮುರಾರ್ಜಿ ದೇಸಾಯಿ ಪರೀಕ್ಷೆ ನಿಮಿತ್ಯ ಕೊಪ್ಪಳ ಜಿಲ್ಲೆಗೆ ಹೋಗಿ ಬಂದಿದ್ದೆ) ತನಗೆ ಅಪರಿಚಿತ ವ್ಯಕ್ತಿ ಒಬ್ಬ ಬಂದು ಪೇಪರ್‌ನಲ್ಲಿ ಹಣವಿಟ್ಟು ತನಗೆ ನೀಡಲು ಬಂದಾಗ ತಾನು ತೆಗೆದುಕೊಳ್ಳಲು ನಿರಾಕರಿಸಿದೆ. ಅಷ್ಟರಲ್ಲಿ ಪೊಲೀಸ್ ಲೋಕಾಯುಕ್ತರು ಬಂದರು ಸದರಿ ಪೇಪರ್ ತೆಗೆದುಕೊಂಡರು ಎಂಬುದಾಗಿ ಹೇಳಿಕೆ ಬರೆದು ಕೊಟ್ಟಿರುತ್ತಾರೆ.

ತನಿಖಾಧಿಕಾರಿಗಳಾದ ಶ್ರೀ ಲಿಂಗಪ್ಪ, ಪೊಲೀಸ್ ಇನ್ಸ್‌ಪೆಕ್ಟರ್, ಕರ್ನಾಟಕ ಲೋಕಾಯುಕ್ತ, ಯಾದಗಿರಿ ಇವರು ಶ್ರೀ ವೆಂಕಯ್ಯ ಇನಾಮಾದಾರ, ಹಿರಿಯ ಸಹಾಯಕ ನಿರ್ದೇಶಕರು ಆಯುಕ್ತರ ಕಛೇರಿ, ಸಾರ್ವಜನಿಕ ಶಿಕ್ಷಣ ಇಲಾಖೆ, ಗುಲ್ಬರ್ಗಾ ಮತ್ತು ಪ್ರಭಾರಿ ಕ್ಷೇತ್ರ ಶಿಕ್ಷಣಾಧಿಕಾರಿ, ಯಾದಗಿರಿ ಇವರ ವಿರುದ್ಧ ದಂಡಾರ್ಹ ಪ್ರಕರಣವನ್ನು ಕರ್ನಾಟಕ ಲೋಕಾಯುಕ್ತ ಯಾದಗಿರಿ ಪೊಲೀಸ್ ಠಾಣೆಯಲ್ಲಿ ಮೊ. ಸಂಖ್ಯೆ : 08/2011 ರಲ್ಲಿ ಲಂಚ ಪ್ರತಿಬಂಧಕ ಕಾಯ್ದೆ 1988ರ ಕಲಂ–7, 13(1)(ಡಿ) ಜೊತೆಯಲ್ಲಿ 13(2)ರ ಅಡಿಯಲ್ಲಿ ದಾಖಲಿಸಿರುತ್ತಾರೆ ಹಾಗೂ ತನಿಖಾಧಿಕಾರಿಗಳಾದ ಶ್ರೀ ತಮ್ಮರಾಯ ಪಾಟೀಲ್, ಆರಕ್ಷಕ ನಿರೀಕ್ಷಕರು, ಕರ್ನಾಟಕ ಲೋಕಾಯುಕ್ತ ಪೊಲೀಸ್ ಠಾಣೆ, ಗುಲ್ಬರ್ಗಾ ಇವರು ಯಾದಗಿರಿ ಲೋಕಾಯುಕ್ತ ಪೊಲೀಸ್ ಠಾಣೆಯಿಂದ ವರ್ಗವಾಗಿ ಬಂದ ದೂರನ್ನು ಗುಲ್ಬರ್ಗಾ ಪೊಲೀಸ್ ಠಾಣೆ ಮೊಕದ್ದಮೆ ಸಂಖ್ಯೆ : 14/2011 (ದಿನಾಂಕ : 1–12–2011) ರಲ್ಲಿ ಲಂಚ ಪ್ರತಿಬಂಧಕ ಕಾಯ್ದೆ 1988ರ ಕಲಂ–7, 13(1)(ಡಿ) ಜೊತೆಯಲ್ಲಿ 13(2)ರ ಅಡಿಯಲ್ಲಿ ದಾಖಲಿಸಿರುತ್ತಾರೆ.

ಆಪಾದಿತರಾದ ಶ್ರೀ ವೆಂಕಯ್ಯ ಇನಾಮದಾರ, ಹಿರಿಯ ಸಹಾಯಕ ನಿರ್ದೇಶಕರು ಆಯುಕ್ತರ ಕಛೇರಿ, ಸಾರ್ವಜನಿಕ ಶಿಕ್ಷಣ ಇಲಾಖೆ, ಗುಲ್ಬರ್ಗಾ ಮತ್ತು ಪ್ರಭಾರಿ ಕ್ಷೇತ್ರ ಶಿಕ್ಷಣಾಧಿಕಾರಿ, ಯಾದಗಿರಿ ಇವರು ಫಿರ್ಯಾದಿದಾರ ಶ್ರೀ ಸದಾಶಿವರೆಡ್ಡಿ ತಂದೆ ಬಸವರಾಜಪ್ಪ ಪಾಟೀಲ್ ಬಿಳ್ಹಾರ, ಶಹಾಪುರ ತಾಲ್ಲೂಕು, ಯಾದಗಿರಿ ಜಿಲ್ಲೆ ಇವರಿಂದ

ಗೊಡಿಹಾಳ ಗ್ರಾಮದ ತುಳಸಿ ಸ್ತ್ರಿ ಶಕ್ತಿ ಸಂಘದ ಅಧ್ಯಕ್ಷರಾದ ಶ್ರೀಮತಿ ಸಿದ್ದಮ್ಮ ಗಂಡ ಮರೆಪ್ಪ ಮತ್ತು ಕಾರ್ಯದರ್ಶಿ ಶ್ರೀಮತಿ ಶರಣಮ್ಮ ಇವರು ಸರ್ಕಾರದಿಂದ ಶಾಲೆಯಿಂದ ಹೊರಗುಳಿದ ಮಕ್ಕಳಿಗಾಗಿ ಗೃಹ ಆಧಾರಿತ ಶಿಕ್ಷಣ ಕಾರ್ಯತಂತ್ರ ಯೋಜನೆ ಮಂಜೂರು ಮಾಡಿಸಿಕೊಂಡು ಬರಲು ಪ್ರಕರಣದ ಫಿರ್ಯಾದಿ ಶ್ರೀ ಸದಾಶಿವರೆಡ್ಡಿ ತಂದೆ ಬಸವರಾಜಪ್ಪ ಪಾಟೀಲ ಇವರಿಗೆ ಕೇಳಿಕೊಂಡಿದ್ದರಿಂದ ಸದರಿ ಶ್ರೀ ಸದಾಶಿವರೆಡ್ಡಿ ಇವರು ಈ ಸ್ತ್ರೀ ಶಕ್ತಿ ಸಂಘದ ಲೆಟರ್ ಪ್ಯಾಡ್‌ನಲ್ಲಿ ಸಂಘದವರ ಸಹಿ ಪಡೆದುಕೊಂಡು ಯಾದಗಿರಿ ಕ್ಷೇತ್ರ ಶಿಕ್ಷಣಾಧಿಕಾರಿಗಳ ಕಛೇರಿಗೆ ಹೋಗಿ ಇನ್ ಚಾರ್ಜ್ ಶಿಕ್ಷಣಾಧಿಕಾರಿಗಳಾದ ಶ್ರೀ ವೆಂಕಯ್ಯ ಇನಾಮಾದಾರ (ಎಜಿಬ) ಇವರಿಗೆ ಭೇಟಿಯಾಗಿ 2011–12ನೇ ಸಾಲಿನ ಗೃಹ ಆಧಾರಿತ ಶಿಕ್ಷಣ ಕಾರ್ಯತಂತ್ರ ಯೋಜನೆ ಮಂಜೂರು ಮಾಡಿಕೊಡಲು ಕೇಳಿಕೊಂಡಾಗ ಸದರಿ ವೆಂಕಯ್ಯ ಇವರು ರೂ. 50,000/– ಲಂಚ ಕೇಳಿದ್ದು ಅದಕ್ಕೆ ಚೌಕಾಸಿ ಮಾಡಿ ರೂ. 30,000/– ಲಂಚ ಕೊಡಲು ಒಪ್ಪಿಕೊಂಡು ಅದರಲ್ಲಿ ರೂ. 22,000/– ಲಂಚದ ಹಣ ಕೊಟ್ಟಾಗ ಅವರು ಇ–ಸ್ಟಾಂಪ್ ಬಾಂಡ್ ಪೇಪರ್ ಮೇಲೆ ಸಹಿ ಮಾಡಿದ್ದು ಒಡಂಬಡಿಕೆ ಪತ್ರದ ಮೇಲೆ ಸಹಿ ಮಾಡಿಕೊಡಲು ಕೇಳಿದಾಗ ಇನ್ನುಳಿದ ಹಣ ಕೊಟ್ಟಾಗ ಸಹಿ ಮಾಡಿಕೊಡುವುದಾಗಿ ಹೇಳಿರುತ್ತಾರೆ. ಒಂದು ತಿಂಗಳ ನಂತರ ಯಾದಗಿರಿ ಕ್ಷೇತ್ರ ಶಿಕ್ಷಣಾಧಿಕಾರಿ ಕಛೇರಿಗೆ ಹೋಗಿ ವಿಚಾರಿಸಿದಾಗ ಬಿಇಒ ಶ್ರೀ ಮಜರ ಹುಸೇನ್ ಇವರು ಸದರಿ ಒಡಂಬಡಿಕೆ ಪತ್ರಕ್ಕೆ ಈ ಹಿಂದೆ ಇನ್–ಚಾರ್ಜ್ ಇದ್ದ ವೆಂಕಯ್ಯ ಇನಾಮಾದಾರ ಇವರೇ ಸಹಿ ಮಾಡಬೇಕಾಗುತ್ತದೆ ಎಂದು ಹೇಳಿದಾಗ ಫಿರ್ಯಾದಿ ಇನಾಮದಾರರವರ ಹತ್ತಿರ ಹೋಗಿ ಒಡಂಬಡಿಕೆ ಪತ್ರಕ್ಕೆ ಸಹಿ ಮಾಡಲು ಕೇಳಿಕೊಂಡಾಗ ರೂ. 5,000/– ಲಂಚದ ಹಣ ಕೊಟ್ಟರೆ ಮಾತ್ರ ಸಹಿ ಮಾಡುವುದಾಗಿ ಹೇಳಿದಾಗ ತನಗೆ ಲಂಚದ ಹಣ ಕೊಡಲು ಮನಸ್ಸಿಲ್ಲದ ಫಿರ್ಯಾದಿದಾರನು ದಿನಾಂಕ : 28–7–2011ರಂದು ಯಾದಗಿರಿ ಲೋಕಾಯುಕ್ತ ಕಛೇರಿಗೆ ಬಂದು ತನಿಖಾಧಿಕಾರಿಯವರಿಗೆ ಮೌಖಿಕವಾಗಿ ಹೇಳಿ ಸ್ವಲಿಖಿತ ದೂರನ್ನು ನೀಡಿರುತ್ತಾರೆ. ದಿನಾಂಕ : 28–7–2011 ರಂದು ಮಧ್ಯಾಹ್ನ 3.00 ಗಂಟೆಗೆ ಆರೋಪಿತ ನೌಕರ ಶ್ರೀ ವೆಂಕಯ್ಯ ತಂದೆ ಬಸವರಾಜ ಇನಾಮಾದಾರ ಶಿಕ್ಷಣಾಧಿಕಾರಿ ಶಿಕ್ಷಣ ಆಯುಕ್ತರ ಕಛೇರಿ ಗುಲ್ಬರ್ಗಾ ಫಿರ್ಯಾದಿಯಾದ ಶ್ರೀ ಸದಾಶಿವರೆಡ್ಡಿ ತಂದೆ ಬಸವರಾಜಪ್ಪ ಪಾಟೀಲ ಸಾ॥ ಬಿಳವಾರ ಇವರಿಂದ ಗೊಡಿಹಾಳ ಗ್ರಾಮದ ತುಳಸಿ ಸ್ತ್ರೀ ಶಕ್ತಿ ಸಂಘದವರು ನಡೆಸುತ್ತಿದ್ದ ಸರ್ಕಾರದಿಂದ ಶಾಲೆಯಿಂದ ಹೊರಗುಳಿದ ಮಕ್ಕಳಿಗಾಗಿ 2011–12ನೇ ಸಾಲಿನ ಗೃಹ ಆಧಾರಿತ ಶಿಕ್ಷಣ ಕಾರ್ಯತಂತ್ರ ಯೋಜನೆ ಮಂಜೂರು ಮಾಡುವ ಸಂಬಂಧ ಒಡಂಬಡಿಕೆ ಪತ್ರದ ಮೇಲೆ ಸಹಿ ಮಾಡಿಕೊಡಲು ಆರೋಪಿತ ನೌಕರನು ಜೇವರ್ಗಿ ಪಟ್ಟಣದ ಟೀಚರ್ಸ್ ಕಾಲೋನಿಯಲ್ಲಿರುವ ತನ್ನ ಮನೆಯಲ್ಲಿ ಫಿರ್ಯಾದಿಯಿಂದ ರೂ. 5,000/– ತೆಗೆದುಕೊಂಡ ನಂತರ ಟ್ರ್ಯಾಪ್ ಮಾಡಿದ್ದು ಸ್ಥಳದಲ್ಲಿಯೇ ಆರೋಪಿತ ನೌಕರನ ಎಡಗೈ ಬೆರಳುಗಳನ್ನು ಸೋಡಿಯಂ ಕಾರ್ಬೋನೇಟ್ ದ್ರಾವಣದಲ್ಲಿ ತೊಳಿಸಿದ್ದಾಗ ದ್ರಾವಣವು ತಿಳಿ ಗುಲಾಬಿ ಬಣ್ಣಕ್ಕೆ ತಿರುಗಿ ಸಕಾರಾತ್ಮಕ ಫಲಿತಾಂಶ ನೀಡಿದ್ದರಿಂದ ಮತ್ತು ಲಂಚದ ಹಣವನ್ನು ಆರೋಪಿತ ನೌಕರನು ಸಹಿ ಮಾಡಲು ಕೊಟ್ಟ ಒಡಂಬಡಿಕೆ ಪತ್ರವನ್ನು ಕೆಳಗಡೆ ಬಿಸಾಕಿದ್ದನ್ನು ನೆರಳು ಸಾಕ್ಷಿದಾರ ಸೂಗುರಪ್ಪನ ಇವರ ಸಹಾಯದಿಂದ ತೆಗೆದುಕೊಂಡು ಲಂಚದ ಹಣ ಜಪ್ತಿ ಮಾಡಿಕೊಂಡಿರುತ್ತದೆ.

ಈ ಎಲ್ಲಾ ಕಾರಣಗಳಿಂದ ಆಪಾದಿತರು ಲಂಚ ನಿರೋಧಕ ಕಾಯ್ದೆ 1988ರ ಕಲಂ–7, 13(1)(ಡಿ) ಜೊತೆಯಲ್ಲಿ ಓದಲಾದ 13(2) ಅಡಿಯಲ್ಲಿ ಶಿಕ್ಷಾರ್ಹ ಅಪರಾಧವನ್ನು ಎಸಗಿರುವುದು ಮೇಲ್ನೋಟಕ್ಕೆ ಮನವರಿಕೆಯಾಗಿದೆ. ಆದ್ದರಿಂದ ಇವರನ್ನು ಲಂಚ ನಿರೋಧಕ ಕಾಯ್ದೆ 1988ರ ಅನ್ವಯ ಕಲಂ–7 13(1)(ಡಿ) ಜೊತೆಯಲ್ಲಿ ಓದಲಾದ 13(2)ರ ಅಡಿಯಲ್ಲಿ ಅಭಿಯೋಜನೆಗೆ ಒಳಪಡಿಸುವುದು ಅವಶ್ಯ ಎಂದು ಸರ್ಕಾರ ಮನಗಂಡಿದೆ.

ಸಕ್ಷಮ ಪ್ರಾಧಿಕಾರವಾದ ಸರ್ಕಾರವು ಆಪಾದಿತರನ್ನು ಕೆಲಸದಿಂದ ವಜಾ ಮಾಡುವ ಅಧಿಕಾರವನ್ನು ಹೊಂದಿದ್ದು, ಲಂಚ ನಿರೋಧಕ ಕಾಯ್ದೆ 1988ರ ಕಲಂ–19(1)(ಬಿ) ರ ಅಡಿ ಆಪಾದಿತ ನೌಕರರಾದ ಶ್ರೀ ವೆಂಕಯ್ಯ ಇನಾಮದಾರ, ಹಿರಿಯ ಸಹಾಯಕ ನಿರ್ದೇಶಕರು ಆಯುಕ್ತರ ಕಛೇರಿ, ಸಾರ್ವಜನಿಕ ಶಿಕ್ಷಣ ಇಲಾಖೆ, ಗುಲ್ಬರ್ಗಾ ಮತ್ತು ಪ್ರಭಾರಿ ಕ್ಷೇತ್ರ ಶಿಕ್ಷಣಾಧಿಕಾರಿ, ಯಾದಗಿರಿ ಇವರನ್ನು ಕಲಂ–7 13(1)(ಡಿ) ಜೊತೆಯಲ್ಲಿ ಓದಲಾದ 13(2)ರ ಅಡಿಯಲ್ಲಿ ದಂಡಾರ್ಹ ಅಪರಾಧ ಎಸಗಿರುವುದರಿಂದ ಸದರಿಯವರನ್ನು ಕಲಂ–19(1)(ಬಿ) ರ ಅಡಿಯಲ್ಲಿ ಸಕ್ಷಮ ನ್ಯಾಯಾಲಯದಲ್ಲಿ ಅಭಿಯೋಜನೆಗೆ ಒಳಪಡಿಸಲು ಸರ್ಕಾರದ ಮಂಜೂರಾತಿ ನೀಡಲು ತೀರ್ಮಾನಿಸಿ ಅದರಂತೆ ಈ ಕೆಳಕಂಡಂತೆ ಆದೇಶ.

**ಸರ್ಕಾರದ ಆದೇಶ ಸಂಖ್ಯೆ : ಇಡಿ 55 ಡಿಜಿಓ 2011, ಬೆಂಗಳೂರು, ದಿನಾಂಕ : 12ನೇ ಫೆಬ್ರವರಿ 2013**

ಪ್ರಸ್ತಾವನೆಯಲ್ಲಿ ವಿವರಿಸಿರುವ ಕಾರಣಗಳ ಹಿನ್ನೆಲೆಯಲ್ಲಿ, ಸರ್ಕಾರವು ಆರೋಪಿಯಾದ ಶ್ರೀ ವೆಂಕಯ್ಯ ಇನಾಮದಾರ, ಹಿರಿಯ ಸಹಾಯಕ ನಿರ್ದೇಶಕರು ಆಯುಕ್ತರ ಕಛೇರಿ, ಸಾರ್ವಜನಿಕ ಶಿಕ್ಷಣ ಇಲಾಖೆ, ಗುಲ್ಬರ್ಗಾ ಮತ್ತು ಪ್ರಭಾರಿ ಕ್ಷೇತ್ರ ಶಿಕ್ಷಣಾಧಿಕಾರಿ, ಯಾದಗಿರಿ ಇವರನ್ನು ಲಂಚ ನಿರೋಧಕ ಕಾಯ್ದೆ 1988ರ ಕಲಂ–7 13(1)(ಡಿ) ಜೊತೆಗೆ 13(2)ರ ಅಡಿಯಲ್ಲಿ ಶಿಕ್ಷಾರ್ಹ ಅಪರಾಧ ಎಸಗಿರುವುದು ದೃಢಪಟ್ಟಿರುವುದರಿಂದ ಸಕ್ಷಮ ನ್ಯಾಯಾಲಯದಲ್ಲಿ ಅಭಿಯೋಗಗೊಳಿಸಲು ಸರ್ಕಾರ ಮಂಜೂರಾತಿಯನ್ನು ನೀಡಿ ಆದೇಶಿಸಿದೆ.

ಮುಂದುವರೆದು, ಕರ್ನಾಟಕ ಸರ್ಕಾರದ (ವ್ಯವಹಾರ) ನಿಯಮಾವಳಿ 1977ರ ನಿಯಮ 18ರ ಪ್ರಕಾರ ಸರ್ಕಾರದ ಪರವಾಗಿ ಅಥವಾ ಸರ್ಕಾರದಿಂದ ಹೊರಡಿಸಲಾಗುವ ಎಲ್ಲಾ ಆದೇಶಗಳನ್ನು ಅಥವಾ ಅಧಿಸೂಚನೆಗಳನ್ನು ಕರ್ನಾಟಕ ಸರ್ಕಾರದ ರಾಜ್ಯಪಾಲರ ಹೆಸರಿನಲ್ಲಿ ಹೊರಡಿಸಬೇಕಿರುತ್ತದೆ.

ಸದರಿ ನಿಯಮಾವಳಿಯ ನಿಯಮ 19(1)(ಬಿ)ರ ಪ್ರಕಾರ ಕರ್ನಾಟಕ ಸರ್ಕಾರದ ರಾಜ್ಯಪಾಲರ ಹೆಸರಿನಲ್ಲಿ ಹೊರಡಿಸಿರುವ ಆದೇಶಗಳು ಮತ್ತು ಅಧಿಸೂಚನೆಗಳು ಒಬ್ಬ ಅಧೀನ ಕಾರ್ಯದರ್ಶಿಯ ಸಹಿಯಿಂದ ಅಧಿಕೃತಗೊಳ್ಳಬೇಕು ಹಾಗೂ ಅಂತಹ ಸಹಿಯು ಅಂತಹ ಆದೇಶ ಅಥವಾ ಲೇಖನವನ್ನು ಸರಿಯಾಗಿ ಅಧಿಕೃತಗೊಳಿಸುತ್ತದೆ.

ಆದ್ದರಿಂದ ಕರ್ನಾಟಕ ಸರ್ಕಾರದ (ವ್ಯವಹಾರ) ನಿಯಮಾವಳಿಗಳು 1977ರ ಈ ಮೇಲ್ಕಂಡ ಆದೇಶವನ್ನು ಸರ್ಕಾರದ ಪರವಾಗಿ ಕಛೇರಿಯ ಮೊಹರು ಮತ್ತು ಸರ್ಕಾರದ ಅಧೀನ ಕಾರ್ಯದರ್ಶಿಯ ಸಹಿಯ ಅಡಿಯಲ್ಲಿ ದಿನಾಂಕ : 12–2–2013ರಂದು ಹೊರಡಿಸಲಾಗಿದೆ.

ಕರ್ನಾಟಕ ರಾಜ್ಯಪಾಲರ ಆದೇಶಾನುಸಾರ ಮತ್ತು ಅವರ ಹೆಸರಿನಲ್ಲಿ

**ಎಸ್.ಬಿ. ಪಟಗಾರ್**

ಸರ್ಕಾರದ ಅಧೀನ ಕಾರ್ಯದರ್ಶಿ,

ಶಿಕ್ಷಣ ಇಲಾಖೆ, (ಸಾಮಾನ್ಯ).

**P.R. 230**

## ಆರ್ಥಿಕ ಸಚಿವಾಲಯ

**ವಿಷಯ :** ಮೀನುಗಾರಿಕೆ ಕ್ಷೇತ್ರಪಾಲಕರಿಗೆ 25 ಮತ್ತು 30 ವರ್ಷಗಳ ಸೇವೆಗೆ ಹೆಚ್ಚುವರಿ ವೇತನ ಬಡ್ತಿ ಮಂಜೂರಾತಿಯಲ್ಲಿ ಕನ್ನಡ ಭಾಷಾ ಪರೀಕ್ಷೆ ಮತ್ತು ಇಲಾಖಾ ಪರೀಕ್ಷೆ ಉತ್ತೀರ್ಣತೆಯಿಂದ ವಿನಾಯಿತಿ ನೀಡುವ ಕುರಿತು.

**ಓದಲಾಗಿದೆ :** ಸರ್ಕಾರಿ ಆದೇಶ ಸಂಖ್ಯೆ : ಆಇ 12 ಎಸ್‌ಆರ್‌ಪಿ 2012 (VIII), ದಿನಾಂಕ : 14ನೇ ಜೂನ್ 2012.

**ಪ್ರಸ್ತಾವನೆ :**

ಮೇಲೆ ಓದಲಾದ ದಿನಾಂಕ : 14–6–2012ರ ಸರ್ಕಾರಿ ಆದೇಶದಲ್ಲಿನ ಆದೇಶ ಭಾಗದ ಕಂಡಿಕೆ 6 (ii) ರಲ್ಲಿ ನಮೂದಿಸಲಾಗಿರುವ ನೌಕರರನ್ನು ಹೊರತುಪಡಿಸಿ ರಾಜ್ಯ ವೇತನ ಶ್ರೇಣಿಗಳ ಮೊದಲ 15 ವೇತನ ಶ್ರೇಣಿಗಳಲ್ಲಿರುವ ಯಾವುದೇ ಒಂದು ಹುದ್ದೆಯಲ್ಲಿ ಇಪ್ಪತ್ತೈದು ವರ್ಷ ಅಥವಾ ಮೂವತ್ತು ವರ್ಷಗಳ ಕಾಲ ಒಂದೂ ಪದೋನ್ನತಿ ಪಡೆಯದೆ ಮುಂದುವರಿದಿರುವ ಅಥವಾ ಮುಂದುವರಿಯುವ ಸರ್ಕಾರಿ ನೌಕರನಿಗೆ ಆ ಹುದ್ದೆಗೆ ನಿಗದಿಪಡಿಸಲಾದ ವೇತನ ಶ್ರೇಣಿಯಲ್ಲಿ ಅಥವಾ ಅವನು ಹೊಂದಿರುವ ಆಯ್ಕೆ ಕಾಲಿಕ ವೇತನ ಶ್ರೇಣಿಯಲ್ಲಿ ಅಥವಾ ಹಿರಿಯ ವೇತನ ಶ್ರೇಣಿಯಲ್ಲಿ ಆಯಾ ಪ್ರಕರಣದನ್ವಯ, 2ನೇ ಹಾಗೂ 3ನೇ ಹೆಚ್ಚುವರಿ ವೇತನ ಬಡ್ತಿಯನ್ನು ದಿನಾಂಕ : 1ನೇ ಏಪ್ರಿಲ್ 2012 ರಿಂದ ಜಾರಿಗೆ ಬರುವಂತೆ ಅಥವಾ 25/30 ವರ್ಷಗಳ ಸೇವೆ ಪೂರ್ಣಗೊಳಿಸಿದ ದಿನಾಂಕದಿಂದ ಇದರಲ್ಲಿ ಯಾವುದು ನಂತರವೋ, ಆ ದಿನಾಂಕದಿಂದ ಮಂಜೂರು ಮಾಡಲು ಆದೇಶಿಸಿರುತ್ತದೆ.

ದಿನಾಂಕ : 14–6–2012ರ ಆದೇಶದನ್ವಯ 2 ಮತ್ತು 3ನೇ ಹೆಚ್ಚುವರಿ ವೇತನ ಬಡ್ತಿಯ ಮಂಜೂರಾತಿ ಉದ್ದೇಶಕ್ಕಾಗಿ ಸರ್ಕಾರಿ ನೌಕರನು ಇತರೆ ಷರತ್ತುಗಳೊಂದಿಗೆ ಮುಂಬಡ್ತಿಗೆ ನಿಗದಿಪಡಿಸಿದ ಅರ್ಹತೆಯನ್ನು ಹೊಂದಿರಬೇಕಾಗುತ್ತದೆ. ಅಂದರೆ ಆ ಹುದ್ದೆಗೆ ನಿಗದಿಪಡಿಸಿದ ಕನ್ನಡ ಭಾಷಾ ಪರೀಕ್ಷೆ ಮತ್ತು ಉನ್ನತ ಹುದ್ದೆಗೆ ಮುಂಬಡ್ತಿ ಹೊಂದಲು ನಿಗದಿಪಡಿಸಿರುವ ಇಲಾಖಾ ಪರೀಕ್ಷೆಗಳಲ್ಲಿ ಸಹ ಸರ್ಕಾರಿ ನೌಕರನು ಉತ್ತೀರ್ಣರಾಗಿಬೇಕಾಗುತ್ತದೆ.

ಮೀನುಗಾರಿಕೆ ಇಲಾಖೆಯ ಮೀನುಗಾರಿಕೆ ಕ್ಷೇತ್ರಪಾಲಕರುಗಳ ನೇಮಕಾತಿಗೆ ಏಳನೇ ತರಗತಿಯಲ್ಲಿ ಉತ್ತೀರ್ಣತೆಯನ್ನು ಕನಿಷ್ಠ ವಿದ್ಯಾರ್ಹತೆಯಾಗಿ ನಿಗದಿಪಡಿಸಲಾಗಿದ್ದು, ಕಡಿಮೆ ವಿದ್ಯಾರ್ಹತೆಯುಳ್ಳ ಈ ನೌಕರರು ಇಲಾಖಾ ಪರೀಕ್ಷೆಗಳಲ್ಲಿ ಉತ್ತೀರ್ಣರಾಗಲು ಅಸಮರ್ಥರಾಗಿರುತ್ತಾರೆ. ವಾರ್ಷಿಕ ವೇತನ ಬಡ್ತಿಗಳಿಸುವ ಉದ್ದೇಶಕ್ಕಾಗಿ ಇವರಿಗೆ ಕನ್ನಡ ಭಾಷಾ ಪರೀಕ್ಷೆ ಉತ್ತೀರ್ಣತೆಯಿಂದ ವಿನಾಯಿತಿ ನೀಡಲಾಗಿರುತ್ತದೆ. ಇದಲ್ಲದೆ ಈ ಹುದ್ದೆಯ ಕಾರ್ಯ ಮತ್ತು ಜವಾಬ್ದಾರಿಗಳು ಪರಿಚಾರಿಕೆ ಸ್ವರೂಪದ್ದಾಗಿದ್ದು, ಮೀನುಮರಿ ಉತ್ಪಾದನೆ, ಮೀನು ಪೋಷಣೆ ಮತ್ತು ಮೀನು ಸಾಕಣೆ, ಕೆರೆಗಳ ಕಾವಲು, ಉಸ್ತುವಾರಿ ಮುಂತಾದ ಕಾರ್ಯಗಳನ್ನು ಒಳಗೊಂಡಿರುತ್ತದೆ. ಈ ಕಾರಣಗಳಿಂದಾಗಿ ಮೀನುಗಾರಿಕೆ ಇಲಾಖೆಯ ಮೀನುಗಾರಿಕೆ ಕ್ಷೇತ್ರಪಾಲಕರಿಗೆ ಕಾಲಬದ್ಧ ಮುಂಬಡ್ತಿ, ಹಿರಿಯ ವೇತನ ಶ್ರೇಣಿ ಮತ್ತು 1ನೇ ಹೆಚ್ಚುವರಿ ವೇತನ ಬಡ್ತಿ ಮಂಜೂರಾತಿಗೆ ಕೂಡ ಆ ಹುದ್ದೆಗೆ ನಿಗದಿಪಡಿಸಿದ ಕನ್ನಡ ಭಾಷಾ ಪರೀಕ್ಷೆಯಲ್ಲಿ ಮತ್ತು ಮುಂಬಡ್ತಿ ಹುದ್ದೆಗೆ ನಿಗದಿಪಡಿಸಿರುವ ಇಲಾಖಾ ಪರೀಕ್ಷೆಗಳಲ್ಲಿ ಉತ್ತೀರ್ಣರಾಗುವುದರಿಂದ ವಿನಾಯಿತಿ ನೀಡಲಾಗಿರುವಂತೆಯೇ 2ನೇ ಮತ್ತು 3ನೇ ಹೆಚ್ಚುವರಿ ವೇತನ ಬಡ್ತಿ ಮಂಜೂರು ಮಾಡುವ ಉದ್ದೇಶಕ್ಕಾಗಿ ಕೂಡ ಆ ಹುದ್ದೆಗೆ ನಿಗದಿಪಡಿಸಿರುವ ಕನ್ನಡ ಭಾಷಾ ಪರೀಕ್ಷೆ ಮತ್ತು ಮುಂಬಡ್ತಿ ಹುದ್ದೆಗೆ ನಿಗದಿಪಡಿಸಿರುವ ಇಲಾಖಾ ಪರೀಕ್ಷೆಗಳ ಉತ್ತೀರ್ಣತೆಯಿಂದ ವಿನಾಯಿತಿ ನೀಡುವಂತೆ ಪಶುಸಂಗೋಪನೆ ಮತ್ತು ಮೀನುಗಾರಿಕೆ ಇಲಾಖೆಯು ಕೋರಿದೆ. ಸರ್ಕಾರವು ಈ ಕೋರಿಕೆಯನ್ನು ಪರಿಶೀಲಿಸಿದೆ.

**ಸರ್ಕಾರಿ ಆದೇಶ ಸಂಖ್ಯೆ : ಆಇ 29 ಎಸ್‌ಆರ್‌ಪಿ 2012, ಬೆಂಗಳೂರು, ದಿನಾಂಕ : 11–2–2013.**

ಮೀನುಗಾರಿಕೆ ಇಲಾಖೆಯ ಮೀನುಗಾರಿಕೆ ಕ್ಷೇತ್ರಪಾಲಕರಿಗೆ ಸರ್ಕಾರಿ ಆದೇಶ ಸಂಖ್ಯೆ : ಆಇ 12 ಎಸ್‌ಆರ್‌ಪಿ 2012 (VIII), ದಿನಾಂಕ: 14–6–2012 ರನ್ವಯ 25 ವರ್ಷಗಳ ಸೇವೆಗಾಗಿ 2ನೇ ಹೆಚ್ಚುವರಿ ವೇತನ ಬಡ್ತಿ ಮತ್ತು 30 ವರ್ಷಗಳ ಸೇವೆಗಾಗಿ 3ನೇ ಹೆಚ್ಚುವರಿ ವೇತನ ಬಡ್ತಿ ಮಂಜೂರು ಮಾಡುವ ಉದ್ದೇಶಕ್ಕಾಗಿ ಆ ಹುದ್ದೆಗೆ ನಿಗದಿಪಡಿಸಿರುವ ಕನ್ನಡ ಭಾಷಾ ಪರೀಕ್ಷೆ ಮತ್ತು ಮುಂಬಡ್ತಿ ಹುದ್ದೆಗೆ ನಿಗದಿಪಡಿಸಿರುವ ಇಲಾಖಾ ಪರೀಕ್ಷೆಗಳ ಉತ್ತೀರ್ಣತೆಗಾಗಿ ಒತ್ತಾಯಿಸುವ ಅಗತ್ಯವಿಲ್ಲವೆಂದು ಸರ್ಕಾರವು ಆದೇಶಿಸಿದೆ.

ಉಳಿದಂತೆ ದಿನಾಂಕ : 14–6–2012 ರ ಆದೇಶದಲ್ಲಿನ ಇತರೆ ಷರತ್ತುಗಳು ಎಂದಿನಂತೆ ಅನ್ವಯಿಸತಕ್ಕದ್ದು.

ಈ ಆದೇಶವು ದಿನಾಂಕ : 1–4–2012 ರಿಂದ ಜಾರಿಗೆ ಬರತಕ್ಕದ್ದು.

ಕರ್ನಾಟಕ ರಾಜ್ಯಪಾಲರ ಆದೇಶಾನುಸಾರ ಮತ್ತು ಅವರ ಹೆಸರಿನಲ್ಲಿ
**ಕೆ.ಎಸ್. ರಾಜಲಕ್ಷ್ಮಿ**
ಸರ್ಕಾರದ ಅಧೀನ ಕಾರ್ಯದರ್ಶಿ,
ಆರ್ಥಿಕ ಇಲಾಖೆ (ಸೇವೆಗಳು–2).

**P.R. 231**

## ಆರ್ಥಿಕ ಸಚಿವಾಲಯ

**ವಿಷಯ :** ಸಮವಸ್ತ್ರ ಭತ್ಯೆ–ದರಗಳ ಪರಿಷ್ಕರಣೆ

**ಓದಲಾಗಿದೆ :** ಸರ್ಕಾರಿ ಆದೇಶ ಸಂಖ್ಯೆ : ಆಇ 12 ಎಸ್‌ಆರ್‌ಪಿ 2012 (III), ದಿನಾಂಕ : 14–6–2012.

**ಸರ್ಕಾರಿ ಆದೇಶ ಸಂಖ್ಯೆ : ಆಇ 3 ಎಸ್‌ಆರ್‌ಪಿ 2013, ಬೆಂಗಳೂರು, ದಿನಾಂಕ : 11ನೇ ಫೆಬ್ರವರಿ, 2013.**

ಮೇಲೆ ಓದಲಾದ ದಿನಾಂಕ: 14–6–2012 ರ ಸರ್ಕಾರಿ ಆದೇಶದಲ್ಲಿನ **"ಪೊಲೀಸ್ ಇಲಾಖೆ"** ಶೀರ್ಷಿಕೆಯಡಿ ಕ್ರಮ ಸಂಖ್ಯೆ : (5)ರ ಕೆಳಗೆ ಈ ನಮೂದುಗಳನ್ನು ಸೇರ್ಪಡೆ ಮಾಡಿಕೊಳ್ಳತಕ್ಕದ್ದು.

| | |
|---|---|
| (6) ಡಿಐಜಿಪಿ (ನಾನ್ ಐಪಿಎಸ್) | ಪ್ರಾರಂಭಿಕವಾಗಿ ರೂ. 4000/–<br>ವರ್ಷಕ್ಕೊಮ್ಮೆ ನವೀಕರಣಕ್ಕಾಗಿ ರೂ. 750/–<br>ನಿರ್ವಹಣಾ ವೆಚ್ಚ ಮಾಸಿಕ ರೂ. 100/– |

ಈ ಆದೇಶವು ತಕ್ಷಣದಿಂದ ಜಾರಿಗೆ ಬರತಕ್ಕದ್ದು.

ಕರ್ನಾಟಕ ರಾಜ್ಯಪಾಲರ ಆದೇಶಾನುಸಾರ ಮತ್ತು ಅವರ ಹೆಸರಿನಲ್ಲಿ
**ಕೆ.ಎಸ್. ರಾಜಲಕ್ಷ್ಮಿ**
ಸರ್ಕಾರದ ಅಧೀನ ಕಾರ್ಯದರ್ಶಿ,
ಆರ್ಥಿಕ ಇಲಾಖೆ (ಸೇವೆಗಳು–2).

## FINANCE SECRETARIAT

**Sub :** Uniform Allowance-Revision of the rates

**Read :** Government Order No. FD 12 SRP 2012 (III), dated : 14-6-2012.

**GOVERNMENT ORDER NO. FD 3 SRP 2013, BANGALORE, DATED : 11TH FEBRUARY 2013.**

In G.O. dated : 14-6-2012 read above, the following entries shall be inserted below Sl.No. (5) under the Heading "POLICE DEPARTMENT".

| | |
|---|---|
| (6) DIGP (Non-IPS) | Initial Grant : Rs. 4000/-<br>Renewal Grant : Rs. 750/- p.a.<br>Maintenance grant Rs. 100/- p.m. |

This order shall come into force with immediate effect.

By Order and in the Name of the Governor of Karnataka,
**K.S. RAJALAKSHMI**
Under Secretary to Government,
Finance Department (Services-2).

**P.R. 232**

## INFORMATION TECHNOLOGY, BIOTECHNOLOGY AND SCIENCE AND TECHNOLOGY SECRETARIAT

**Sub :** Setting-up of Agri Biotech Park on PPP mode in UAS, Dharwad campus-Constitution of Steering Committee-Orders reg.

**Preamble :**

The Department has initiated steps for setting-up an Agri Biotech Park on PPP mofe in the campus of University of Agricultural Sciences, Dharwad. M/s. Ernst and Young have been engaged by M/s. Karnataka Biotechnology and Information Technology Services (KBITS) for the said Project as Management Consultants.

A round of discussion was held by Principal Secretary, Department of IT, BT and S & T, with Principal Secretary, Department of Agriculture, in the chambers of the latter on 16th November, 2012. Various aspects of the Agri Biotech Park were discussed along with the role envisaged for UAS, Dharwad in the project. In the said meeting, it was decided to constitute a Steering Committee under the Chairmanship of Principal Secretary, Department of IT, BT and S & T, for suggesting the steps required to be taken for speedy implementation of the Agri Biotech Park project. Members of the Steering Committee were also suggested during the meeting. Hence the Order :

**GOVERNMENT ORDER NO. ITD 05 MDA 2012, BANGALORE, DATED : 21-12-2012**

In the circumstances explained above, Government hereby constitute a Steering Committee for the proposed Agri Biotech Park project in UAS, Dharwad.

| | | | |
|---|---|---|---|
| 1. | Principal Secretary, Department of IT, BT and S & T, Government of Karnataka | - | Chairman |
| 2. | Vice Chancellor, University of Agricultural Sciences, Dharwad | - | Member |
| 3. | Shri Vasanth Kumar, Additional Secretary, Department of Agriculture, Government of Karnataka | - | Member |
| 4. | Representative of Ernst & Young, PMC | - | Member |
| 5. | Dr. Krishnaraj, Head of the Department, Institute of Agri Biotechnology, UAS, Dharwad | - | Member |
| 6. | Director, IT and BT and Managing Director, KBITS | - | Member Secretary. |

The Steering Committee would also examine the RFP and other documents prepared by the Project Management Consultants and suggest necessary steps for the successful implementation of the project.

By Order and in the Name of the Governor of Karnataka,
**E. RAMAKRISHNAPPA**
Under Secretary to Government,
Information Technology, Biotechnology and Science and Technology Department.

**P.R. 233**

